KA / BG-GPO / 2515 / WPP-47 / 2009-2011

# ಕರ್ನಾಟಕ ರಾಜ್ಯಪತ್ರ

ಅಧಿಕೃತವಾಗಿ ಪ್ರಕಟಿಸಲಾದುದು

| ಸಂಪುಟ ೧೪೪ | ಬೆಂಗಳೂರು, ಗುರುವಾರ, ಆಗಸ್ಟ್ ೧೩, ೨೦೦೯ (ಶ್ರಾವಣ ೨೨, ಶಕ ವರ್ಷ ೧೯೩೧) | ಸಂಚಿಕೆ ೩೩ |
|---|---|---|

## ಭಾಗ – ೧

## ರಾಜ್ಯ ಸರ್ಕಾರದ ಮುಖ್ಯ ಆದೇಶಗಳು ಹಾಗೂ ಸುತ್ತೋಲೆ ಮುಂತಾದ ಎಲ್ಲಾ ಇಲಾಖೆಗಳಿಗೂ ಸಂಬಂಧಿಸಿದ ಆದೇಶಗಳು

**ಒಳಾಡಳಿತ ಸಚಿವಾಲಯ**

**ವಿಷಯ:** ಶ್ರೀ ಜಿ.ಎಚ್.ನಂಜುಂಡಸ್ವಾಮಿ, ಎ.ಎಸ್.ಐ., ಸದಾಶಿವನಗರ ಸಂಚಾರ ಪೊಲೀಸ್ ಠಾಣೆ, ಬೆಂಗಳೂರು ನಗರ, ಇವರು ಸರ್ಕಾರಕ್ಕೆ ಸಲ್ಲಿಸಿರುವ ಪರಿಷ್ಕರಣ ಮೇಲ್ಮನವಿ ಅರ್ಜಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:**
1) ಶಿಸ್ತು ಪ್ರಾಧಿಕಾರಿ ಹಾಗೂ ಡೆಪ್ಯೂಟಿ ಪೊಲೀಸ್ ಕಮೀಷನರ್, ಸಂಚಾರ ಪೂರ್ವ ವಿಭಾಗ, ಬೆಂಗಳೂರು ನಗರ, ಇವರ ಆದೇಶ ಸಂಖ್ಯೆ:ಇವಿ/2/ಆರ್/–6/ಡಿಸಿಪಿ/ಸಂ.ಪೊ.2006 ದಿ:07.05.2007.
2) ಮೇಲ್ಮನವಿ ಪ್ರಾಧಿಕಾರಿ ಹಾಗೂ ಅಡಿಷನಲ್ ಪೊಲೀಸ್ ಕಮೀಷನರ್, ಸಂಚಾರ, ಬೆಂಗಳೂರು ನಗರ, ಇವರ ಆದೇಶ ಸಂಖ್ಯೆ:45/ಅಪೀಲು/ 2007 ದಿನಾಂಕ:09–02–2008.
3) ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ:22–04–2008.
4) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)13/2008–09 ದಿ:20–02–2009.

**ಪ್ರಸ್ತಾವನೆ:–**

ಶ್ರೀ ಜಿ.ಎಚ್.ನಂಜುಂಡಸ್ವಾಮಿ, ಎ.ಎಸ್.ಐ., ಸದಾಶಿವನಗರ ಸಂಚಾರ ಪೊಲೀಸ್ ಠಾಣೆ, ಬೆಂಗಳೂರು ನಗರ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಇವರು ಹಲಸೂರು ಗೇಟ್ ಪೊಲೀಸ್ ಠಾಣೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ ಕರ್ತವ್ಯಲೋಪವೆಸಗಿ ದುರ್ನಡತೆ ಮತ್ತು ಬೇಜವಾಬ್ದಾರಿತನ ಪ್ರದರ್ಶಿಸಿದ ಕಾರಣದ ಮೇಲೆ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿಗಳು) ನಿಯಮಾವಳಿ 1965ರ ನಿಯಮ 7 ರಡಿ ಈ ಕೆಳಕಂಡಂತೆ ದೋಷಾರೋಪಣೆ ಯನ್ನು ಹೊರಿಸಲಾಗಿತ್ತು.

**ದೋಷರೋಪಣೆ:–**

"ಶ್ರೀ ಜಿ.ಎಚ್.ನಂಜುಂಡಸ್ವಾಮಿ, ಆದ ನೀವು ಹಲಸೂರುಗೇಟ್ ಸಂಚಾರ ಪೊಲೀಸ್ ಠಾಣೆಯಲ್ಲಿ ಎ.ಎಸ್.ಐ. ಆಗಿ ಕರ್ತವ್ಯವನ್ನು ನಿರ್ವಹಿಸುತ್ತಿದ್ದು, ದಿ:26–10–2006 ರಂದು ರಾತ್ರಿ ಸುಮಾರು 9–20 ಗಂಟೆಯ ಸಮಯದಲ್ಲಿ ಸದಾಶಿವನಗರ 9ನೇ ಮುಖ್ಯ ರಸ್ತೆ, 5ನೇ ಅಡ್ಡರಸ್ತೆ ಜಂಕ್ಷನ್ ಬಳಿ ಇನೋವ ಕಾರ್ ನಂ.ಕೆಎ–03 ಎಂಎ–6369ರ ಚಾಲಕ ವಾಹನವನ್ನು ಅತೀ ಜೋರಾಗಿ ಚಾಲನೆ ಮಾಡಿಕೊಂಡು ಬಂದು ಕೆಎ–04 ಇಎನ್–1007 ಮತ್ತು ಕೆಎ–4 ಇಎನ್–2729ರ ಸವಾರರಿಗೆ ಡಿಕ್ಕಿ ಮಾಡಿದ್ದು, ಕೆಎ–04 ಇಎನ್–1007ರ ಸವಾರ ಶ್ರೀ ವಾಸುದೇವ್, ರವರು ಮೃತಪಟ್ಟಿದ್ದು, ಕೆಎ–4 ಇಎನ್–2729ರ ಸವಾರ ಮತ್ತು ಹಿಂಬದಿ ಸವಾರರು ತೀವ್ರ ರಕ್ತಗಾಯಗೊಂಡಿರುತ್ತಾರೆ. ಈ ಸಂಬಂಧ ನಿಯಂತ್ರಣ ಕೋಣೆಯಿಂದ ಬಂದ ಸಂದೇಶದ ಮೇರೆಗೆ ಅಪಘಾತ ಸಂಭವಿಸಿದ ಸ್ಥಳಕ್ಕೆ ಹೋಗಿ ನೋಡುವಂತೆ ಸೂಚನೆ ಬಂದಿದ್ದು,

ಅದರಂತೆ ನೀವು ಅಪಘಾತ ಸ್ಥಳಕ್ಕೆ ಹೋಗಿ ಅಪಘಾತದ ಬಗ್ಗೆ ಪರಿಶೀಲಿಸಿ ಮೃತ ಮತ್ತು ಗಾಯಾಳುಗಳನ್ನು ಅಪಘಾತ ಸ್ಥಳದಿಂದ ಸಾರ್ವಜನಿಕರ ಸಹಾಯದೊಂದಿಗೆ ಎಂ.ಎಸ್.ರಾಮಯ್ಯ ಆಸ್ಪತ್ರೆಗೆ ಸಾಗಿಸಿದ್ದು, ನಂತರ ಆರೋಪಿ ಇನೋವಾ ವಾಹನದ ಚಾಲಕ ಶ್ರೀ ಬಿ.ಜೆ.ಸಂಗೀತ, ರವರನ್ನು ನೋಡಿ ಅವರೊಂದಿಗೆ ಮಾತನಾಡಿದ್ದು, ಸದರಿ ಆರೋಪಿಯನ್ನು ದಸ್ತಗಿರಿ ಮಾಡುವ ಯಾವುದೇ ಪ್ರಯತ್ನವನ್ನು ಮಾಡದೇ ನಂತರ ಅಪಘಾತದ ಸ್ಥಳಕ್ಕೆ ಬಂದು ಆರೋಪಿ ತಲೆ ತಪ್ಪಿಸಿಕೊಳ್ಳಲು ಅನುವು ಮಾಡಿಕೊಟ್ಟಿರುತ್ತೀರಿ. ಹಾಗೂ ಪ್ರಕರಣದ ತನಿಖಾಧಿಕಾರಿಗಳಿಗೆ ಸದರಿ ಆರೋಪಿ ಕಾರ್ ಚಾಲಕನ ಬಗ್ಗೆ ಸೂಕ್ತ ಮಾಹಿತಿಯನ್ನು ನೀಡದೇ ಹಾಗೂ ವಿಚಾರವನ್ನು ಸರಿಯಾಗಿ ತಿಳಿಸದೆ ವಿಷಯವನ್ನು ಮರೆಮಾಚಿ ಶಿಸ್ತಿನ ಇಲಖೆಯ ಒಬ್ಬ ಜವಾಬ್ದಾರಿಯುತ ಅಧಿಕಾರಿಯಾದ ನೀವು ಶಿಸ್ತಿನ ಇಲಾಖೆಗೆ ಸಲ್ಲದ ರೀತಿಯಲ್ಲಿ ವರ್ತಿಸಿ ಅಧಿಕಾರವನ್ನು ದುರುಪಯೋಗಪಡಿಸಿಕೊಂಡು ಶಿಸ್ತಿನ ಇಲಾಖೆಯಲ್ಲಿ ಅಶಿಸ್ತನ್ನು ಪ್ರದರ್ಶಿಸಿ, ಕರ್ತವ್ಯ ಲೋಪವೆಸಗಿ ದುರ್ನಡತೆ ಮತ್ತು ಬೇಜವಾಬ್ದಾರಿತನವನ್ನು ಪ್ರದರ್ಶಿಸಿರುತ್ತೀರಿ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರಿ ಹಾಗೂ ಉಪಪೊಲೀಸ್ ಅಯುಕ್ತರು, ಸಂಚಾರ ಪೂರ್ವವಲಯ, ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 07–05–2007ರ ಆದೇಶದಲ್ಲಿ ಅರ್ಜಿದಾರರ "ಇವರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ತದನಂತರದ ವೇತನ ಬಡ್ತಿ ಗಳಿಗೆ ದಕ್ಕೆಯಾಗದಂತೆ ಆರು ತಿಂಗಳ ಕಾಲ ಮುಂದೂಡುವ ದಂಡನೆಯನ್ನು ವಿಧಿಸಿ ದಿ:31–10–06 ರಿಂದ 18–12–06ರ ವರೆಗಿನ ಅಮಾನತ್ತಿನ ಅವಧಿಯನ್ನು ಅಮಾನತ್ತೆಂದೆ ಪರಿಗಣಿಸಿ ಆದೇಶಿಸಿದ್ದಾರೆ."

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಅಡಿಷನಲ್ ಕಮೀಷನರ್, ಸಂಚಾರ, ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ:(2)ರಲ್ಲಿ ಓದಲಾದ ದಿನಾಂಕ:09.02.2008ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನೂ, ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಪರಿಷ್ಕರಣ ಮೇಲ್ಮನವಿಯಲ್ಲಿ ಪರಿಗಣಿಸುವಂತಹ ಯಾವುದೇ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಅತೀವ ನಿರ್ಲಕ್ಷತೆ, ದುರ್ನಡತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ, ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವೆಂದು ಪರಿಗಣಿಸುತ್ತಾ, ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಒಇ 63 ಪೊಸಿಅ 2009 ಬೆಂಗಳೂರು, ದಿನಾಂಕ: 18ನೇ ಏಪ್ರಿಲ್ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಜಿ.ಎಚ್.ನಂಜುಂಡಸ್ವಾಮಿ, ಎ.ಎಸ್.ಐ., ಸದಾಶಿವನಗರ ಸಂಚಾರ ಪೊಲೀಸ್ ಠಾಣೆ, ಬೆಂಗಳೂರು ನಗರ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1314

**ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ಟಿ.ಎಸ್.ತಿರುಮಲಯ್ಯ, ಪೊಲೀಸ್ ಸಬ್–ಇನ್ಸ್‌ಪೆಕ್ಟರ್, ಮಾಜಿ ಪ್ರಧಾನ ಮಂತ್ರಿಗಳ ಕುಟುಂಬ ಭದ್ರತೆ, ಬೆಂಗಳೂರು, ಇವರು ಸರ್ಕಾರಕ್ಕೆ ಸಲ್ಲಿಸಿರುವ ಪರಿಷ್ಕರಣ ಮೇಲ್ಮನವಿ ಅರ್ಜಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:**
1) ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ತುಮಕೂರು, ಇವರ ಆದೇಶ ಸಂಖ್ಯೆ:ಪನ್ಸಿ/90/2007–08 ಓ.ಬಿ:90/2008 ದಿ:13–02–2008
2) ಮೇಲ್ಮನವಿ ಪ್ರಾಧಿಕಾರಿ ಹಾಗೂ ಆರಕ್ಷಕ ಮಹಾ ನಿರೀಕ್ಷಕರು, ಕೇಂದ್ರ ವಲಯ, ಬೆಂಗಳೂರು, ಇವರ ಆದೇಶ ಸಂಖ್ಯೆ:ಅಪೀಲು 3/2008–09 ಓ.ಬಿ.ಸಂ:32/2008–09 ದಿನಾಂಕ:27–05–08
3) ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ:01–12–2008
4) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)99/2008–09 ದಿ:06–03–2009

**ಪ್ರಸ್ತಾವನೆ:–**

ಶ್ರೀ ಟಿ.ಎಸ್. ತಿರುಮಲಯ್ಯ, ಪೊಲೀಸ್ ಸಬ್–ಇನ್ಸ್‌ಪೆಕ್ಟರ್, ಮಾಜಿ ಪ್ರಧಾನ ಮಂತ್ರಿಗಳ ಕುಟುಂಬ ಭದ್ರತೆ, ಬೆಂಗಳೂರು, (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಇವರು ಚಿಕ್ಕಮಗಳೂರು ಗ್ರಾಮಾಂತರ ಪೊಲೀಸ್ ಠಾಣೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿರುವಾಗ ಕರ್ತವ್ಯದಲ್ಲಿ ನಿರ್ಲಕ್ಷತನ ಕರ್ತವ್ಯಲೋಪ ಮತ್ತು ದುರ್ನಡತೆ ಪ್ರದರ್ಶಿಸಿರುವ ಕಾರಣದ ಮೇಲೆ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿಗಳು) ನಿಯಮಾವಳಿ 1965ರ ನಿಯಮ 7 ರಡಿ ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿತ್ತು.

**ದೋಷರೋಪಣೆ:–**

> "ಚಿಕ್ಕಮಗಳೂರು ಗ್ರಾಮಾಂತರ ಪೊಲೀಸ್ ಠಾಣಾ ವ್ಯಾಪ್ತಿಯ ಬ್ಯಾರವಳ್ಳಿ ಗ್ರಾಮದ ಸ.ನಂ.308/2ರ ಆಸ್ತಿಯಲ್ಲಿನ ಸಿಲ್ವರ್ ಮರದ ಕಟಾವಿನ ವಿಚಾರವಾಗಿ ಶ್ರೀ ಶಶಿಧರ ಹಾಗೂ ಶ್ರೀ ರಮೇಶ್, ರವರಿಂದ ಅಕ್ರಮ ಸಂಭಾವನೆಯನ್ನು ಪಡೆದು, ನಿಯಮಬಾಹಿರವಾಗಿ ಸಿಲ್ವರ್ ಮರಗಳನ್ನು ತುಂಬಿಕೊಂಡು ಹೋಗಲು ಸಹಕಾರ ನೀಡಿ ನಿಮ್ಮ ಕರ್ತವ್ಯದಲ್ಲಿ ನಿರ್ಲಕ್ಷತೆ ಮತ್ತು ಕರ್ತವ್ಯಲೋಪ ಮತ್ತು ದುರ್ನಡತೆಯನ್ನು ತೋರಿರುತ್ತೀರಿ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ತುಮಕೂರು, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 13–02–08ರ ಆದೇಶದಲ್ಲಿ "ಇವರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ತದನಂತರದ ವಾರ್ಷಿಕ ವೇತನ ಬಡ್ತಿಗಳ ಮೇಲೆ ಪರಿಣಾಮ ಬೀರದಂತೆ 6 ತಿಂಗಳ ಕಾಲ ಮುಂದೂಡುವ ದಂಡನೆಯನ್ನು ವಿಧಿಸಿದ್ದಾರೆ."

ಈ ಆದೇಶದ ವಿರುದ್ದ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಆರಕ್ಷಕ ಮಹಾ ನಿರೀಕ್ಷಕರು, ಕೇಂದ್ರ ವಲಯ, ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ:(2)ರಲ್ಲಿ ಓದಲಾದ ದಿನಾಂಕ:27–05–08ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು, ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಸಾಕ್ಷ್ಯಾಧಾರಗಳ ಆಧಾರದ ಮೇಲೆ ಶಿಸ್ತುಪ್ರಾಧಿಕಾರವು ದಂಡನೆಯನ್ನು ವಿಧಿಸಿದ್ದು, ಪರಿಷ್ಕರಣ ಮೇಲ್ಮನವಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಅತೀವ ನಿರ್ಲಕ್ಷತೆ, ದುರ್ನಡತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ, ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವೆಂದು ಪರಿಗಣಿಸುತ್ತಾ, ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಒಇ 381 ಪೊಸಿಅ 2008 ಬೆಂಗಳೂರು, ದಿನಾಂಕ: 18ನೇ ಏಪ್ರಿಲ್ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಟಿ.ಎಸ್.ತಿರುಮಲಯ್ಯ, ಪೊಲೀಸ್ ಸಬ್–ಇನ್ಸ್‌ಪೆಕ್ಟರ್, ಮಾಜಿ ಪ್ರಧಾನ ಮಂತ್ರಿಗಳ ಕುಟುಂಬ ಭದ್ರತೆ, ಬೆಂಗಳೂರು, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1315

**ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ಉಮೇಶ್, ಸಿ.ಪಿ.ಸಿ.–66, ಡಿ.ಎ.ಆರ್., ಉಡುಪಿ ಜಿಲ್ಲೆ, ಇವರು ಸರ್ಕಾರಕ್ಕೆ ಸಲ್ಲಿಸಿರುವ ಪರಿಷ್ಕರಣ ಮೇಲ್ಮನವಿ ಅರ್ಜಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:**
1) ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಉಡುಪಿ, ಇವರ ಆದೇಶ ಸಂಖ್ಯೆ:ಸಿಬ್ಬಂದಿ(3)03/ಇವಿ/ಉಜಿ:2005 ದಿ:03–01–07
2) ಮೇಲ್ಮನವಿ ಪ್ರಾಧಿಕಾರಿ ಹಾಗೂ ಇನ್ಸ್‌ಪೆಕ್ಟರ್ ಜನರಲ್ ಆಫ್ ಪೊಲೀಸ್, ಪಶ್ಚಿಮ ವಲಯ, ಮಂಗಳೂರು, ಇವರ ಆದೇಶ ಸಂಖ್ಯೆ:ಸಿಬ್ಬಂದಿ 2/ಮೇಲ್ಮನವಿ/05–2007 ದಿನಾಂಕ:16–06–08
3) ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ:22–09–2008
4) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ:ಅಪೀಲು(2)71/2008–09 ದಿನಾಂಕ:11–03–2007

**ಪ್ರಸ್ತಾವನೆ:–**

ಶ್ರೀ ಉಮೇಶ್, ಸಿ.ಪಿ.ಸಿ.–66, ಡಿ.ಎ.ಆರ್., ಉಡುಪಿ ಜಿಲ್ಲೆ, (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಇವರು ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತನ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿದ ಹಿನ್ನೆಲೆಯಲ್ಲಿ ಇತರೇ 3 ಸಿಬ್ಬಂದಿಗಳ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿಗಳು) ನಿಯಮಾವಳಿ 1965ರ ನಿಯಮ 6 ಮತ್ತು 8 ರಡಿ ಜಂಟಿ ಇಲಾಖಾ ವಿಚಾರಣೆಗೆ ಆದೇಶಿಸಿ, ಈ ಕೆಳಕಂಡ ದೋಷಾರೋಪಣೆಯನ್ನು ಹೊರಿಸಲಾಗಿತ್ತು.

**ದೋಷರೋಪಣೆ:–**

> "ಉಡುಪಿ ಜಿಲ್ಲಾ ಸರ್ಕಾರಿ ಆಸ್ಪತ್ರೆಯಲ್ಲಿರುವ ಖೈದಿ ಸಿರಾಜ್ ಹಸನ್‌ನ ಕಾವಲು ಕರ್ತವ್ಯಕ್ಕೆ ಶ್ರೀ.ಉಮೇಶ, ಎ.ಪಿ.ಸಿ.–66, ಡಿ.ಎ.ಆರ್. ಉಡುಪಿ ಆದ ನಿಮ್ಮನ್ನು ನೇಮಿಸಲಾಗಿದ್ದು, ಸದ್ರಿ ಖೈದಿಗೆ ಹೊರಗಿನಿಂದ ಆಹಾರ, ಬಿಸ್ಲರಿ ಕಂಪನಿಗೆ ಸೇರಿದ ಮಿನರಲ್ ವಾಟರ್, ಸಿಗರೇಟು, ಮೊಬೈಲ್ ಪೋನ್ ಬಳಕೆ, ಇತ್ಯಾದಿ ಸವಲತ್ತುಗಳನ್ನು ನೀಡಿದ್ದಲ್ಲದೇ, ವೀಕ್ಷಕರಿಗೆ ಯಾವುದೇ ಅನುಮತಿ ಇಲ್ಲದೇ ಖೈದಿಯನ್ನು ನೋಡಲು ಅನುವು ಮಾಡಿಕೊಟ್ಟಿದ್ದು, ದಿ:02–04–05 ರಂದು ಸಮಯ ಸುಮಾರು 15–30 ಗಂಟೆಗೆ ಖೈದಿ ಸಿರಾಜ್ ಹಸನ್, ನಿಮ್ಮ ಸುಪರ್ದಿಯಿಂದ ತಪ್ಪಿಸಿಕೊಂಡು ಹೋಗಲು ಕಾರಣರಾಗಿ ಖೈದಿ ಭದ್ರಿಕೆ ಕಾವಲು ಕರ್ತವ್ಯದಲ್ಲಿ ತೀವ್ರ ರೀತಿಯ ನಿರ್ಲಕ್ಷತನ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿ ಕರ್ತವ್ಯಲೋಪ ವೆಸಗಿರುವ ಆರೋಪಣೆ."

ಮೇಲ್ಕಂಡ ಆರೋಪದ ಮೇಲೆ ಇಲಾಖಾ ವಿಚಾರಣೆ ನಡೆಸಿ, ವಿಚಾರಣಾಧಿಕಾರಿಗಳು ಆರೋಪವನ್ನು ಎರಡು ಭಾಗವಾಗಿ ಪರಿಶೀಲಿಸಿ (2)ನೇ ಭಾಗವಾದ ವಿಚಾರಣಾಧೀನ ಖೈದಿಯು ತಪ್ಪಿಸಿಕೊಂಡು ಹೋಗಲು ಕಾರಣರಾಗಿರುವ ಆರೋಪವು ಸಾಬೀತಾಗಿದೆ ಎಂದು ಅಭಿಪ್ರಾಯ ಪಟ್ಟಿರುವ ವರದಿ ಆಧಾರದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಉಡುಪಿ, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ:03–01–2007ರ ಆದೇಶದಲ್ಲಿ ``ಅರ್ಜಿದಾರರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ತದನಂತರದ ವೇತನ ಬಡ್ತಿಗೆ ದಕ್ಕೆಯಾಗುವಂತೆ 3 ವರ್ಷಗಳ ಕಾಲ ತಡೆಹಿಡಿದು ದಿ:04–04–2005 ರಿಂದ 23–07–05ರ ವರೆಗಿನ ಅಮಾನತ್ತಿನ ಅವಧಿಯನ್ನು ಅಮಾನತ್ತೆಂದೇ ಪರಿಗಣಿಸುವ ದಂಡನೆಯನ್ನು ವಿಧಿಸಿದ್ದಾರೆ.``

ಈ ಆದೇಶದ ವಿರುದ್ದ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಇನ್ಸ್‌ಪೆಕ್ಟರ್ ಜನರಲ್ ಆಫ್ ಪೊಲೀಸ್, ಪಶ್ಚಿಮ ವಲಯ, ಮಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ:(2)ರಲ್ಲಿ ಓದಲಾದ ದಿನಾಂಕ: 16–06–08ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನೂ, ಇಲಾಖಾ ವಿಚಾರಣೆ ದಾಖಲೆಗಳನ್ನು ಪರಿಶೀಲಿಸಲಾಗಿದೆ. ಪರಿಷ್ಕರಣ ಮೇಲ್ಮನವಿಯನ್ನು ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಅತೀವ ನಿರ್ಲಕ್ಷತೆ, ದುರ್ನಡತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ, ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವೆಂದು ಪರಿಗಣಿಸುತ್ತಾ, ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಒಇ 310 ಪೊಸಿಅ 2008 ಬೆಂಗಳೂರು, ದಿನಾಂಕ: 18ನೇ ಏಪ್ರಿಲ್ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ.ಉಮೇಶ್, ಎ.ಪಿ.ಸಿ.–66, ಡಿ.ಎ.ಆರ್. ಉಡುಪಿ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1316 **ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ಸಿ.ಸಿ.ಪಾಟೀಲ್, ಪಿ.ಐ., ತಿಪಟೂರು ನಗರ ಪೊಲೀಸ್ ಠಾಣೆ, ತುಮಕೂರು, ಇವರು ಸರ್ಕಾರಕ್ಕೆ ಸಲ್ಲಿಸಿರುವ ಪರಿಷ್ಕರಣ ಮೇಲ್ಮನವಿ ಅರ್ಜಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:**
1) ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ತುಮಕೂರು, ಇವರ ಆದೇಶ ಸಂಖ್ಯೆ:ಪನ್ಸಿ/28/2007–08 ಓ.ಬಿ:583/07 ದಿ:13–12–2007
2) ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಕೇಂದ್ರ ವಲಯ, ಬೆಂಗಳೂರು, ಇವರ ಆದೇಶ ಸಂಖ್ಯೆ:ಅಪೀಲು 70/2007–08 ಓ.ಬಿ.ಸಂ:28/2007 ದಿನಾಂಕ:23–05–08

3) ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ:22–07–2008

4) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಸಿಬಿ(8)49/2008–09 ದಿ:18–02–2009

**ಪ್ರಸ್ತಾವನೆ:–**

ಶ್ರೀ ಸಿ.ಸಿ.ಪಾಟೀಲ್, ಪಿ.ಐ., ತಿಪಟೂರು ನಗರ ಪೊಲೀಸ್ ಠಾಣೆ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಇವರು ಕರ್ತವ್ಯದಲ್ಲಿ ನಿರ್ಲಕ್ಷತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿದ ಕಾರಣದ ಮೇಲೆ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿಗಳು) ನಿಯಮಾವಳಿ 1965ರ ನಿಯಮ 7 ರಡಿ ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷರೋಪಣೆ:–**

"ಮುಲ್ಕಿ ಇರುವ ಅರ್ಜಿಗಳ ಬಗ್ಗೆ ವಿಚಾರಣೆ ನಡೆಸಿ ವಿಚಾರಣಾ ವರದಿಯನ್ನು ಸಲ್ಲಿಸಲು ಡಿವೈ.ಎಸ್.ಪಿ., ತಿಪಟೂರು ಉಪ ವಿಭಾಗ, ರವರು ಮೌಖಿಕವಾಗಿ, ಮಾಸಿಕ ಸಭೆಯಲ್ಲಿ ಮತ್ತು ಜ್ಞಾಪನ ಪತ್ರಗಳ ಮೂಲಕ ತಿಳಿಸಿದ್ದರೂ ಸಹ ನೀವು ಮುಲ್ಕಿ ಇರುವ ಅರ್ಜಿಗಳ ಬಗ್ಗೆ ವಿಚಾರಣೆ ನಡೆಸಿ ವರದಿಯನ್ನು ಸಲ್ಲಿಸಲು ವಿಫಲರಾಗಿ ನಿಮ್ಮ ಕರ್ತವ್ಯದಲ್ಲಿ ನಿರ್ಲಕ್ಷತೆ ಹಾಗೂ ಬೇಜವಾಬ್ದಾರಿ ತನ ತೋರಿರುತ್ತೀರಿ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಕೋರಿದ್ದು, ನಿಗದಿತ ಅವಧಿಯಲ್ಲಿ ಸಮಜಾಯಿಷಿಯನ್ನು ನೀಡದೆ ಇದ್ದುದರಿಂದ ಸಾಕ್ಷ್ಯಾಧಾರಗಳ ಮೇಲೆ ಶಿಸ್ತುಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ತುಮಕೂರು, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ:13–12–2007ರ ಆದೇಶದಲ್ಲಿ ``ಇವರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ತದನಂತರದ ವಾರ್ಷಿಕ ವೇತನ ಬಡ್ತಿಗೆ ದಕ್ಕೆಯಾಗದಂತೆ ಆರು ತಿಂಗಳ ಕಾಲ ಮುಂದೂಡುವ ದಂಡನೆಯನ್ನು ವಿಧಿಸಿದ್ದಾರೆ."

ಈ ಆದೇಶದ ವಿರುದ್ದ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಕೇಂದ್ರ ವಲಯ, ಬೆಂಗಳೂರು, ಇವರು ಕ್ರಮ ಸಂಖ್ಯೆ:(2)ರಲ್ಲಿ ಓದಲಾದ ದಿನಾಂಕ:23.05.2008ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನೂ, ಇಲಾಖಾ ವಿಚಾರಣೆ ದಾಖಲೆಗಳನ್ನು ಪರಿಶೀಲಿಸಲಾಗಿದೆ. ಪರಿಷ್ಕರಣ ಮೇಲ್ಮನವಿಯಲ್ಲಿ ಪರಿಗಣಿಸುವಂತಹ ಯಾವುದೇ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ನಿರ್ಲಕ್ಷತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ, ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವೆಂದು ಪರಿಗಣಿಸುತ್ತಾ, ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಒಇ 217 ಪೊಸಿಅ 2008 ಬೆಂಗಳೂರು, ದಿನಾಂಕ: 18ನೇ ಏಪ್ರಿಲ್ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ.ಸಿ.ಸಿ.ಪಾಟೀಲ್, ಪಿ.ಐ., ತಿಪಟೂರು ನಗರ ಪೊಲೀಸ್ ಠಾಣೆ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1317

**ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ಎ.ಡಿ.ಬಸಣ್ಣವರ, ಪೊಲೀಸ್ ಇನ್ಸ್‌ಪೆಕ್ಟರ್, ಬ್ರಹ್ಮಪುರ ಪೊಲೀಸ್ ಠಾಣೆ, ಗುಲ್ಬರ್ಗಾ, ಇವರು ಸರ್ಕಾರಕ್ಕೆ ಸಲ್ಲಿಸಿರುವ ಪರಿಷ್ಕರಣ ಮೇಲ್ಮನವಿ ಅರ್ಜಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:** 1) ಶಿಸ್ತು ಪ್ರಾಧಿಕಾರಿ ಹಾಗೂ ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಆದೇಶ ಸಂಖ್ಯೆ:ಸಿಬಿ(5) 53/2005–06 ದಿ:12–07–2006

2) ಅರ್ಜಿದಾರರ ಮೇಲ್ಮನವಿ ಅರ್ಜಿ ದಿನಾಂಕ:19–05–2007

3) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಸಿಬಿ(8)84/2005–06 ದಿ:04–06–2007

**ಪ್ರಸ್ತಾವನೆ:–**

ಶ್ರೀ ಎ.ಡಿ.ಬಸಣ್ಣವರ, ಪೊಲೀಸ್ ಇನ್ಸ್‌ಪೆಕ್ಟರ್, ಬ್ರಹ್ಮಪುರ ಪೊಲೀಸ್ ಠಾಣೆ, ಗುಲ್ಬರ್ಗಾ, (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಇವರು ಕಮರಿಪೇಟೆ ಪೊಲೀಸ್ ಠಾಣೆ, ಹುಬ್ಬಳ್ಳಿ–ಧಾರವಾಡ ಇಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ ಕರ್ತವ್ಯದಲ್ಲಿ ಬೇಜವಾಬ್ದಾರಿತನ, ಅಶಿಸ್ತು ಮತ್ತು ನಿರ್ಲಕ್ಷತೆ ಪ್ರದರ್ಶಿಸಿದ ಕಾರಣದ ಮೇಲೆ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿಗಳು) ನಿಯಮಾವಳಿ 1965ರ ನಿಯಮ 7 ರಡಿ ಈ ಕೆಳಕಂಡಂತೆ ದೋಷಾರೋಪಣೆ ಯನ್ನು ಹೊರಿಸಲಾಗಿದೆ.

**ದೋಷರೋಪಣೆ:–**

> "ನೀವು ಹಿಂದೆ ಪಿ.ಐ.ಆಗಿ ಕಮರಿಪೇಟೆ ಪೊಲೀಸ್ ಠಾಣೆ, ಹುಬ್ಬಳ್ಳಿ–ಧಾರವಾಡ ಇಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ ನೀವು ದಿ:22–08–05 ರಂದು ನ್ಯಾಯಾಲಯದ ಕರ್ತವ್ಯದ ಮೇಲೆ ಗುಲ್ಬರ್ಗಾ ಜಿಲ್ಲೆಗೆ ಹೋಗಿದ್ದು, ನಂತರ ಬಂದು ಕರ್ತವ್ಯಕ್ಕೆ ವರದಿ ಮಾಡಿಕೊಳ್ಳದೆ, ಈ ಕಛೇರಿಯ ಆದೇಶ ಸಂಖ್ಯೆ:ಸಿಬಿ(2)114/ 2005–06, ದಿ:21.01.2006ರಲ್ಲಿ ನಿಮ್ಮನ್ನು ಖಾನಾಪುರ ವೃತ್ತ, ಬೆಳಗಾವಿ ಜಿಲ್ಲೆಗೆ ವರ್ಗಾವಣೆ ಮಾಡಿದ್ದು, ನೀವು ಪೊಲೀಸ್ ಆಯುಕ್ತರು, ಹುಬ್ಬಳ್ಳಿ–ಧಾರವಾಡ ರವರಿಂದ ಕರ್ತವ್ಯದಿಂದ ಬಿಡುಗಡೆ ಹೊಂದದೆ, ನೇರವಾಗಿ ವರ್ಗಾವಣೆಯಾದ ಸ್ಥಳಕ್ಕೆ ವರದಿ ಮಾಡಿಕೊಂಡು ಕರ್ತವ್ಯದಲ್ಲಿ ದುರ್ನಡತೆ, ಬೇಜವಾಬ್ದಾರಿತನ, ಅಶಿಸ್ತು ಮತ್ತು ನಿರ್ಲಕ್ಷತೆ ಎಸಗಿರುತ್ತೀರಿ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರಿ ಹಾಗೂ ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ:12–07–2006ರ ಆದೇಶದಲ್ಲಿ "ಅರ್ಜಿದಾರರ ಮುಂದಿನ ಒಂದು ವಾರ್ಷಿಕ ವೇತನ ಬಡ್ತಿಯನ್ನು ತದನಂತರದ ವೇತನ ಬಡ್ತಿಗಳ ಮೇಲೆ ಪರಿಣಾಮ ಬೀರದಂತೆ ಒಂದು ವರ್ಷಕಾಲ ಮುಂದೂಡುವ ದಂಡನೆಯನ್ನು ವಿಧಿಸಿರುತ್ತಾರೆ "

ಈ ಆದೇಶದ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನೂ, ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಪರಿಷ್ಕರಣ ಮೇಲ್ಮನವಿಯಲ್ಲಿ ಯಾವುದೇ ಹೊಸ ಸಮರ್ಥನೀಯ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಅತೀವ ನಿರ್ಲಕ್ಷತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ, ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವೆಂದು ಪರಿಗಣಿಸುತ್ತಾ, ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಒಇ 155 ಪೊಸಿಅ 2007 ಬೆಂಗಳೂರು, ದಿನಾಂಕ: 7ನೇ ಮೇ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ.ಎ.ಡಿ.ಬಸಣ್ಣವರ, ಪೊಲೀಸ್ ಇನ್ಸ್‌ಪೆಕ್ಟರ್, ಬ್ರಹ್ಮಪುರ ಪೊಲೀಸ್ ಠಾಣೆ, ಗುಲ್ಬರ್ಗಾ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1361

**ಟಿ.ಎನ್.ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ಪಿ.ಸೀನಪ್ಪ, ಮಾಜಿ ಎ.ಪಿ.ಸಿ.–1584, ಸಿ.ಎ.ಆರ್.(ದಕ್ಷಿಣ) ಬೆಂಗಳೂರು, ಇವರು ಸರ್ಕಾರಕ್ಕೆ ಸಲ್ಲಿಸಿರುವ ಪರಿಷ್ಕರಣ ಮೇಲ್ಮನವಿ ಅರ್ಜಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:**
1) ಶಿಸ್ತು ಪ್ರಾಧಿಕಾರಿ ಹಾಗೂ ಉಪ ಪೊಲೀಸ್ ಆಯುಕ್ತರು, ನಗರ ಸಶಸ್ತ್ರ ಮೀಸಲು ಪಡೆ, ದಕ್ಷಿಣ ಬೆಂಗಳೂರು, ಇವರ ಆದೇಶ ಸಂಖ್ಯೆ:ಡಿಇ:7:ಆರ್–6/2005–06 ದಿನಾಂಕ:23–02–2005
2) ಮೇಲ್ಮನವಿ ಪ್ರಾಧಿಕಾರಿ ಹಾಗೂ ಜಂಟಿ ಪೊಲೀಸ್ ಆಯುಕ್ತರು, ಸಿ.ಎ.ಆರ್. ಬೆಂಗಳೂರು, ಇವರ ಆದೇಶ ಸಂಖ್ಯೆ:07/ಅಪೀಲು/2006 ದಿ:18–07–2005
3) ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ:31–08–2007
4) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)78/2007–08 ದಿ:04–11–2007
5) ಕರ್ನಾಟಕ ಲೋಕ ಸೇವಾ ಆಯೋಗದ ಪತ್ರ ಸಂಖ್ಯೆ:ಪಿಎಸ್‌ಸಿ 116 ಸಿಎನ್‌ಎಸ್ 08 ದಿನಾಂಕ:18.03.2009

**ಪ್ರಸ್ತಾವನೆ:–**

ಶ್ರೀ ಪಿ.ಸೀನಪ್ಪ, ಮಾಜಿ ಎ.ಪಿ.ಸಿ.–1584, ಸಿ.ಎ.ಆರ್.(ದಕ್ಷಿಣ) ಬೆಂಗಳೂರು, (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ದಿ:05–12–2004 ರಿಂದ 05–07–2005ರ ವರೆಗೆ ಅನಧಿಕೃತವಾಗಿ ಗೈರುಹಾಜರಾದ ಹಿನ್ನೆಲೆಯಲ್ಲಿ ಇವರ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಿಯಮಗಳು) ನಿಯಮಾವಳಿ 1965ರ ನಿಯಮ 6ರಡಿ ಇಲಾಖಾ ವಿಚಾರಣೆಗೆ ಆದೇಶಿಸಿ, ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷರೋಪಣೆ:–**

"ಆರಕ್ಷಕ ಪೇದೆ 1584, ಸೀನಪ್ಪ ಎಚ್ ಪಂಗಡ, ಸಿ.ಎ.ಆರ್, ದಕ್ಷಿಣ, ಆಡುಗೋಡಿ, ಬೆಂಗಳೂರು, ಆದ ನೀವು ದಿ:05–12–2004 ರಿಂದ ಯಾವುದೇ ಪೂರ್ವಾನುಮತಿಯನ್ನು ಪಡೆಯದೆ ಹಾಗೂ ಯಾವುದೇ ರಜೆ ಮಂಜೂರಾತಿಯನ್ನು ಪಡೆಯದೆ ಮತ್ತು ಯಾವುದೇ ವಿಧದಲ್ಲಿಯೂ ನಿಮ್ಮ ಗೈರುಹಾಜರಿಯ ಕಾರಣವನ್ನು ಮುಂಗಡವಾಗಿ ಕಛೇರಿಗೆ ತಿಳಿಸದೆ ಇಲಾಖಾ ನಿಯಮ ಉಲ್ಲಂಘಿಸಿ, ಕರ್ತವ್ಯಕ್ಕೆ ಅನಧಿಕೃತವಾಗಿ ಗೈರು ಹಾಜರಾಗಿ, ಗೈರುಹಾಜರಿಯಲ್ಲಿಯೇ ಮುಂದುವರಿದಿರುತ್ತೀರಿ. ಇದು ಶಿಸ್ತಿನ ಇಲಾಖೆಯಲ್ಲಿ ಸೇವೆ ಸಲ್ಲಿಸುತ್ತಿರುವ ನಿಮ್ಮ ಅಶಿಸ್ತು ದುರ್ನಡತೆ ಹಾಗೂ ಬೇಜವಾಬ್ದಾರಿಯನ್ನು ತೋರಿಸುತ್ತದೆ."

ಮೇಲ್ಕಂಡ ಆರೋಪದ ಮೇಲೆ ಇಲಾಖಾ ವಿಚಾರಣೆ ನಡೆಸಿ, ವಿಚಾರಣಾಧಿಕಾರಿಗಳು ಆರೋಪ ಸಾಬೀತಾಗಿದೆ ಎಂದು ಸಲ್ಲಿಸಿದ ವರದಿ ಆಧಾರದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರಿ ಹಾಗೂ ಉಪ ಪೊಲೀಸ್ ಆಯುಕ್ತರು, ನಗರ ಸಶಸ್ತ್ರ ಮೀಸಲು ಪಡೆ, ದಕ್ಷಿಣ ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ:(1) ರಲ್ಲಿ ಓದಲಾದ ದಿನಾಂಕ: 23–02–2005ರ ಆದೇಶದಲ್ಲಿ "ಇವರನ್ನು ಸೇವೆಯಿಂದ ವಜಾಗೊಳಿಸಿ ದಿ:05–12–2004 ರಿಂದ 05–07–2005ರ ವರೆಗಿನ ಅನಧಿಕೃತವಾಗಿ ಗೈರುಹಾಜರಾದ ಅವಧಿ ಯನ್ನು ವೇತನರಹಿತ ರಜೆ ಎಂದು ಪರಿಗಣಿಸಿ ಆದೇಶಿಸಿದ್ದಾರೆ."

ಈ ಆದೇಶದ ವಿರುದ್ದ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಜಂಟಿ ಪೊಲೀಸ್ ಆಯುಕ್ತರು, ಸಿ.ಎ.ಆರ್. ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ:(2) ರಲ್ಲಿ ಓದಲಾದ ದಿನಾಂಕ:18.07.2005ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನೂ, ಇಲಾಖಾ ವಿಚಾರಣೆ ದಾಖಲೆಗಳನ್ನು ಪರಿಶೀಲಿಸಲಾಗಿದೆ. ಅರ್ಜಿದಾರರು ಸೇವೆಗೆ ಅನಧಿಕೃತವಾಗಿ ಗೈರು ಹಾಜರಾಗಿರುವುದು ಸಾಬೀತಾಗಿದ್ದು, ಅನಾರೋಗ್ಯದ ಕಾರಣ ನೀಡಿರುವುದನ್ನು ಸರ್ಕಾರವು ಮಾನವೀಯ ದೃಷ್ಠಿಯಿಂದ ಪರಿಗಣಿಸಿ ಶಿಸ್ತುಪ್ರಾಧಿಕಾರದ ದಂಡನಾದೇಶವನ್ನು ಭಾಗಶ: ಮಾರ್ಪಡಿಸಲು ತೀರ್ಮಾನಿಸಿ, ಈ ಕುರಿತು ಕರ್ನಾಟಕ ಲೋಕಸೇವಾ ಆಯೋಗದ ಸಹಮತಿಯನ್ನು ಓದಲಾದ (5)ರ ಪತ್ರದಲ್ಲಿ ಪಡೆದು, ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಒಇ 49 ಪೊಸಿಅ 2008 ಬೆಂಗಳೂರು, ದಿನಾಂಕ: 29ನೇ ಏಪ್ರಿಲ್ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25 ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಪಿ.ಸೀನಪ್ಪ, ಮಾಜಿ ಎ.ಪಿ.ಸಿ.–1584, ಸಿ.ಎ.ಆರ್.(ದಕ್ಷಿಣ) ಬೆಂಗಳೂರು, ಇವರಿಗೆ ಶಿಸ್ತುಪ್ರಾಧಿಕಾರ ವಿಧಿಸಿದ ದಂಡನಾದೇಶವನ್ನು ಮಾರ್ಪಡಿಸಿ, ಇವರನ್ನು ಸೇವೆಯಿಂದ ವಜಾಗೊಳಿಸಿ ಹೊರಡಿಸಿದ ಶಿಸ್ತುಪ್ರಾಧಿಕಾರಿಯ ದಿ:23–12–05ರ ಆದೇಶದ ದಿನಾಂಕದಿಂದಲೇ ಜಾರಿಗೆ ಬರುವಂತೆ ಕಡ್ಡಾಯ ನಿವೃತ್ತಿಗೊಳಿಸಿ ಆದೇಶಿಸಿದೆ. ಇವರು ಕರ್ತವ್ಯಕ್ಕೆ ಅನಧಿಕೃತವಾಗಿ ಗೈರುಹಾಜರಾದ ಅವಧಿಯಾದ ದಿ:05–12–2004 ರಿಂದ 05–07–2005ರ ವರೆಗಿನ ಅವಧಿ ಯನ್ನು ಅಸಾಧಾರಣ ರಜೆಯೆಂದು ಪರಿಗಣಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1362

**ಟಿ.ಎನ್.ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ರಮೇಶ, ಮಾಜಿ ಸಿಪಿಸಿ–315, ಚಾಮರಾಜನಗರ ಗ್ರಾಮೀಣ ಪೊಲೀಸ್ ಠಾಣೆ, ಚಾಮರಾಜನಗರ ಜಿಲ್ಲೆ, ಇವರು ಸರ್ಕಾರಕ್ಕೆ ಸಲ್ಲಿಸಿರುವ ಪರಿಷ್ಕರಣ ಮೇಲ್ಮನವಿ ಅರ್ಜಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:**

1) ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಚಾಮರಾಜನಗರ ಜಿಲ್ಲೆ, ಇವರ ಆದೇಶ ಸಂಖ್ಯೆ:ಡಿಇ 01/2006–07 ಓ.ಬಿ:92/2007 ದಿನಾಂಕ:15–06–2007
2) ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ದಕ್ಷಿಣ ವಲಯ, ಮೈಸೂರು, ಇವರ ಆದೇಶ ಸಂಖ್ಯೆ:ಅಪೀಲು 40/2007–08 ದಿ:20–01–2008

3) ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ:02–04–08

4) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)23/2008–09 ದಿ:25–07–2008

5) ಕರ್ನಾಟಕ ಲೋಕ ಸೇವಾ ಆಯೋಗದ ಪತ್ರ ಸಂಖ್ಯೆ:ಪಿಎಸ್‌ಸಿ 164 ಸಿಎನ್‌ಎಸ್ 08 ದಿನಾಂಕ:01.04.2009

**ಪ್ರಸ್ತಾವನೆ:–**

ಶ್ರೀ ರಮೇಶ, ಮಾಜಿ ಸಿಪಿಸಿ–315, ಚಾಮರಾಜನಗರ ಜಿಲ್ಲೆ, ಗ್ರಾಮಾಂತರ ಪೊಲೀಸ್ ಠಾಣೆಯಲ್ಲಿ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯ ನಿರ್ವಹಿಸುತ್ತಿದ್ದಾಗ ದುರ್ನಡತೆಯ ಕಾರಣದ ಮೇಲೆ ಇವರ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಿಯಮಗಳು) ನಿಯಮಾವಳಿ 1965ರ ನಿಯಮ 6ರಡಿ ಇಲಾಖಾ ವಿಚಾರಣೆಗೆ ಆದೇಶಿಸಿ, ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷರೋಪಣೆ:–**

"ಕುಮಾರಿ ಎಂ.ಸವಿತ ಬಿನ್ ಎಂ.ಮಂಚಯ್ಯ, 28ವರ್ಷ, ಪರಿಶಿಷ್ಟ ಜನಾಂಗ, ಅಂಚೆ ಕಛೇರಿ ಪಕ್ಕ, ಮುಸ್ಲೀಂ ಬೀದಿ, ಯಳಂದೂರು ಪಟ್ಟಣ ಇವರು ದಿ:14–02–2006 ರಂದು ಯಳಂದೂರು ಪೊಲೀಸ್ ಠಾಣೆಗೆ ಹಾಜರಾಗಿ ನಿಮ್ಮ ವಿರುದ್ಧ ಫಿರ್ಯಾದನ್ನು ನೀಡಿ ದಿ:14–02–2006ರ ಹಿಂದಿನ ದಿನಗಳಲ್ಲಿ ರಮೇಶ್, ಸಿಪಿಸಿ–315 ಆದ ನೀವು ಫಿರ್ಯಾದು ದಾರರನ್ನು ಮದುವೆ ಮಾಡಿಕೊಳ್ಳುತ್ತೇನೆಂದು ನಂಬಿಸಿ ಫಿರ್ಯಾದುದಾರರ ಜೊತೆಯಲ್ಲಿ ಬಲವಂತವಾಗಿ ಸಂಭೋಗ ನಡೆಸಿದ್ದು, ಈಗ ಫಿರ್ಯಾದು ದಾರರನ್ನು ಮದುವೆಯಗುವುದಿಲ್ಲ, ಈ ವಿಚಾರ ಯಾರಿಗಾದರೂ ತಿಳಿಸಿದರೆ ಫಿರ್ಯಾದುದಾರರನ್ನು ಕೊಲೆ ಮಾಡುತ್ತೇನೆಂದು ಕೊಲೆ ಬೆದರಿಕೆ ಹೂಡಿರುತ್ತೀರೆಂದು, ಆರೋಪಿಸಿದ ಮೇರೆಗೆ ನಿಮ್ಮ ವಿರುದ್ಧ ಯಳಂದೂರು ಪೊಲೀಸ್ ಠಾಣೆ ಮೊ.ಸಂ:10:2006 ಕಲಂ 376, 493, 506 ರೀತ್ಯಾ ಪ್ರಕರಣದ ದಾಖಲಾಗಿರುತ್ತದೆ.

ಶ್ರೀ ರಮೇಶ, ಸಿಪಿಸಿ–315 ಚಾಮರಾಜನಗರ ಗ್ರಾಮಂತರ ಠಾಣೆ ಆದ ನಿಮ್ಮ ಸೇವಾ ಪುಸ್ತಕವನ್ನು ಪರಿಶೀಲಿಸಲಾಗಿ ನಿಮಗೆ ಈಗಾಗಲೆ ಮದುವೆಯಾಗಿದ್ದು ನಿಮ್ಮ ಪತ್ನಿಯ ಹೆಸರು ಶ್ರೀಮತಿ. ರಮ್ಯ ಆಗಿರುತ್ತದೆ. ನೀವು ಮದುವೆಯಾಗಿದ್ದರೂ ಬೇರೊಬ್ಬ ಮಹಿಳೆಯನ್ನು ಮದುವೆಯಾಗುತ್ತೇನೆಂದು ನಂಬಿಸಿ ಆಕೆಯೊಂದಿಗೆ ಬಲತ್ಕಾರದಿಂದ ಸಂಭೋಗ ನಡೆಸಿ, ಆಕೆಯನ್ನು ವಂಚಿಸಿ ಕೊಲೆ ಬೆದರಿಕೆಯೊಡ್ಡಿ ಶಿಸ್ತಿನ ಇಲಾಖೆಗೆ ಅಗೌರವ ತರುವ ರೀತಿಯಲ್ಲಿ ಅಸಭ್ಯವಾಗಿ ದುರ್ನಡತೆ ಪ್ರದರ್ಶಿಸಿ ಕ್ರಿಮಿನಲ್ ಮೊಕದ್ದಮೆಯಲ್ಲಿ ಆರೋಪಿಯಾಗಿ ಭಾಗವಹಿಸಿರುತ್ತೀರಿ."

ಮೇಲ್ಕಂಡ ಆರೋಪದ ಮೇಲೆ ಇಲಾಖಾ ವಿಚಾರಣೆ ನಡೆಸಿ, ವಿಚಾರಣಾಧಿಕಾರಿಗಳು ಆರೋಪ ಸಾಬೀತಾಗಿದೆ ಎಂದು ಸಲ್ಲಿಸಿದ ವರದಿ ಆಧಾರದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಚಾಮರಾಜನಗರ ಜಿಲ್ಲೆ, ಇವರು ಮೇಲೆ ಕ್ರಮ ಸಂಖ್ಯೆ: (1) ರಲ್ಲಿ ಓದಲಾದ ದಿನಾಂಕ:15.06.2007ರ ಆದೇಶದಲ್ಲಿ ಅರ್ಜಿದಾರರರನ್ನು ಸೇವೆಯಿಂದ ವಜಾಗೊಳಿಸಿ, ಅಮಾನತ್ತಿನ ಅವಧಿಯನ್ನು ಜೀವನ ಭತ್ಯೆಗೆ ಮಿತಗೊಳಿಸುವ ದಂಡನೆಯನ್ನು ವಿಧಿಸಿರುತ್ತಾರೆ.

ಈ ಆದೇಶದ ವಿರುದ್ದ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ದಕ್ಷಿಣ ವಲಯ, ಮೈಸೂರು, ಇವರು ಮೇಲೆ ಕ್ರಮ ಸಂಖ್ಯೆ:(2) ರಲ್ಲಿ ಓದಲಾದ ದಿನಾಂಕ:20–01–2008 ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನೂ, ಇಲಾಖಾ ವಿಚಾರಣೆ ದಾಖಲೆಗಳನ್ನು ಪರಿಶೀಲಿಸಲಾಗಿದೆ. ಅರ್ಜಿದಾರರ ವಿರುದ್ಧದ ಆರೋಪವು ಸಾಬೀತಾಗಿದ್ದರೂ ದಂಡನೆಯು ಅರ್ಜಿದಾರರ ಕುಟುಂಬದ ಹಿತದೃಷ್ಟಿಯಿಂದ ಪರಿಶೀಲಿಸಿದಾಗ ಸ್ವಲ್ಪ ಮಟ್ಟಿಗೆ ಹೆಚ್ಚಿನದಾಗಿ ಕಂಡು ಬಂದಿರುವುದರಿಂದ ಈ ಕುರಿತು ಕರ್ನಾಟಕ ಲೋಕಸೇವಾ ಆಯೋಗದ ಸಹಮತಿಯನ್ನು ಓದಲಾದ (5)ರ ಪತ್ರದಲ್ಲಿ ಪಡೆದು, ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಒಇ 309 ಪೊಸಿಅ 2008 ಬೆಂಗಳೂರು, ದಿನಾಂಕ: 29ನೇ ಏಪ್ರಿಲ್ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25 ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ.ರಮೇಶ, ಮಾಜಿ ಸಿಪಿಸಿ–315, ಚಾಮರಾಜನಗರ ಜಿಲ್ಲೆ, ಗ್ರಾಮಾಂತರ ಪೊಲೀಸ್ ಠಾಣೆ, ಇವರಿಗೆ ಶಿಸ್ತುಪ್ರಾಧಿಕಾರವು ವಿಧಿಸಿದ ದಂಡನಾದೇಶವನ್ನು ಮಾರ್ಪಡಿಸಿ, ಇವರನ್ನು ಸೇವೆಯಿಂದ ವಜಾಗೊಳಿಸಿ, ಶಿಸ್ತುಪ್ರಾಧಿಕಾರ ಹೊರಡಿಸಿದ ದಿ:15–06–2007ರ ಆದೇಶದ ದಿನಾಂಕದಿಂದಲೇ ಜಾರಿಗೆ ಬರುವಂತೆ ಕಡ್ಡಾಯ ನಿವೃತ್ತಿಗೊಳಿಸಿ ಆದೇಶಿಸಿದೆ. ಇವರ ಅಮಾನತ್ತಿನ ಅವಧಿಯನ್ನು ಅಮಾನತ್ತೆಂದು ಪರಿಗಣಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1363

**ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ಎಂ.ಎ.ನಟರಾಜ್, ಪಿ.ಐ., ಸಾಗರ ಪೊಲೀಸ್ ಠಾಣೆ, ಶಿವಮೊಗ್ಗ ಜಿಲ್ಲೆ, ಇವರು ಸರ್ಕಾರಕ್ಕೆ ಸಲ್ಲಿಸಿರುವ ಪರಿಷ್ಕರಣ ಮೇಲ್ಮನವಿ ಅರ್ಜಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:** 1) ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಚಿಕ್ಕಮಗಳೂರು ಇವರ ಆದೇಶ ಸಂಖ್ಯೆ:ಸಿಆರ್/76/2001 ದಿನಾಂಕ:26–09–2001

2) ಅರ್ಜಿದಾರರ ಮೇಲ್ಮನವಿ ಅರ್ಜಿ ದಿನಾಂಕ:11–03–2008

3) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ:ಸಿಬಿ(8) 02/2008–09 ದಿ:23–03–2009

**ಪ್ರಸ್ತಾವನೆ:–**

ಶ್ರೀ ಎಂ.ಎ.ನಟರಾಜ್, ಪಿ.ಐ., ಸಾಗರ ಪೊಲೀಸ್ ಠಾಣೆ, ಇವರು ಚಿಕ್ಕಮಗಳೂರು ನಗರ ಪೊಲೀಸ್ ಠಾಣೆಯಲ್ಲಿ ಪೊಲೀಸ್ ಸಬ್–ಇನ್ಸ್‌ಪೆಕ್ಟರ್ ಅಗಿ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತೆ ಮತ್ತು ಬೇಜವಾಬ್ದಾರಿತನ ಪ್ರದರ್ಶಿಸಿದ ಕಾರಣದ ಮೇಲೆ ಇವರ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿಗಳು) ನಿಯಮಾವಳಿ 1965ರ ನಿಯಮ 7ರಡಿ ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷರೋಪಣೆ:–**

1. ಶ್ರೀ ಎಂ.ಎ.ನಟರಾಜ್, ನೀವು ನಗರ ಪೊಲೀಸ್ ಠಾಣೆಯಲ್ಲಿ ಪೊಲೀಸ್ ಉಪ ನಿರೀಕ್ಷಕರಾಗಿ ಕರ್ತವ್ಯ ನಿರ್ವಹಿಸಿಕೊಂಡಿದ್ದೀರಿ. ಠಾಣಾ ಬರಹಗಾರರಾದ ಸಿ.ಎಚ್.ಸಿ.–60, ಟಿ.ಎಂ.ರಾಜಣ್ಣ, ರವರು ಠಾಣಾ ಸಿಬ್ಬಂದಿಗಳ ಪ್ರತಿ ತಿಂಗಳ ಆರ್.ಡಿ. ಹಣದ ಬಾಬ್ತು ಆಯಾಯಾ ತಿಂಗಳೇ ಅಂಚೆ ಕಛೇರಿಗೆ ಪಾವತಿಸದೆ ದುರುಪಯೋಗಪಡಿಸಿಕೊಳ್ಳುತ್ತಿದ್ದಾಗ್ಯೂ ನೀವು ಗಮನಹರಿಸದೆ ಆಲಕ್ಷಮಾಡಿ ಠಾಣಾ ಬರಹಗಾರರ ಅಕ್ರಮ ಚಟುವಟಿಕೆಗೆ ಪರೋಕ್ಷವಾಗಿ ಕಾರಣರಾಗಿದ್ದೀರಿ.
2. ಠಾಣಾ ಬರಹಗಾರರು ಠಾಣಾ ಸಿಬ್ಬಂದಿಗಳ ವಾರದ ರಜಾಭತ್ಯೆ ಹಣವನ್ನು ಹಾಗೂ ಪ್ರಯಾಣಭತ್ಯೆ ಹಣವನ್ನು ಸಿಬ್ಬಂದಿಗಳಿಗೆ ಸಂಪೂರ್ಣವಾಗಿ ವಿತರಿಸದೇ ವಿತರಣೆಯ ಸಮಯದಲ್ಲಿ ಈ ಹಣದಲ್ಲಿ ಭಾಗಾಂಶ ವನ್ನು ಪಡೆದು ಸಿಬ್ಬಂದಿಗಳಿಗೆ ಮೋಸ ಮಾಡುತ್ತಿದ್ದಾಗ್ಯೂ ನೀವು ಗಮನಹರಿಸದೆ ಠಾಣಾ ಬರಹಗಾರರ ದಿನಂಪ್ರತಿ ಅಕ್ರಮ ಚಟುವಟಿಕೆಯ ಕಡೆ ಲಕ್ಷವಿರದೆ ಅತೀವ ನಿರ್ಲಕ್ಷತೆ ಬೇಜವಾಬ್ದಾರಿ ಯನ್ನು ಪ್ರದರ್ಶಿಸಿರುತ್ತೀರಿ.”

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಚಿಕ್ಕಮಗಳೂರು, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ:26–09–2001ರ ಆದೇಶದಲ್ಲಿ “ಅರ್ಜಿದಾರರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ತದನಂತರದ ವೇತನ ಬಡ್ತಿಗೆ ದಕ್ಕೆಯಾಗದಂತೆ ಮೂರು ತಿಂಗಳ ಕಾಲ ಮುಂದೂಡುವ ದಂಡನೆ ವಿಧಿಸಿರುತ್ತಾರೆ.”

ಈ ಆದೇಶದ ವಿರುದ್ಧ ಮೇಲ್ಮನವಿ ಪ್ರಾಧಿಕಾರಕ್ಕೆ ಮೇಲ್ಮನವಿಯನ್ನು ಸಲ್ಲಿಸದೆ ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿಯನ್ನು ಸಲ್ಲಿಸಿದ್ದಾರೆ.

ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನೂ, ದಾಖಲೆಗಳನ್ನಾಗಿ ಪರಿಶೀಲಿಸಲಾಗಿದೆ. ಪರಿಷ್ಕರಣ ಮೇಲ್ಮನವಿಯಲ್ಲಿ ಪರಿಗಣಿಸಬಹುದಾದಂತಹ ಯಾವುದೇ ಸಮರ್ಥನೀಯ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ನಿರ್ಲಕ್ಷತೆ, ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ.

ಆದ್ದರಿಂದ, ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವೆಂದು ಪರಿಗಣಿಸುತ್ತಾ, ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಒಇ 96 ಪೊಸಿಅ 2009 ಬೆಂಗಳೂರು, ದಿನಾಂಕ: 29ನೇ ಮೇ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಎಂ.ಎ. ನಟರಾಜ್, ಪಿ.ಐ., ಸಾಗರ ಪೊಲೀಸ್ ಠಾಣೆ, ಶಿವಮೊಗ್ಗ ಜಿಲ್ಲೆ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1424

**ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**FOREST, ECOLOGY AND ENVIRONMENT SECRETARIAT**

**Sub:** Diversion of 8.79 ha. of forest land for construction of 33 KV DC line from Muthinakoppa Substation to N.R.Pura Substation and N.R.Pura Substation to Koppa Substation in N.R.Pura Taluk, Chickmagtalur District in favour of Executive Engineer(Elect.,) MESCOM Ltd., Chickmagalur.

**Read:**
1. Letter No.A5(4)GFL.CR.27/03-04, dated 24-03-2006 of Principal Chief Conservator of Forests, Bangalore.
2. State Government letter No.FEE 56 FGL 2006, dated :20.07.2006.
3. Letter No. F©A/11.2/279/KAR/TL/130, dated 25-05-2007 of Government of India, Ministry of Environment and Forests, Regional Office, (South Zone), Bangalore.
4. Letter No.A5(4)GFL.CR.27/03-04,dated 04-09-2008 of Principal Chief Conservator of Forests, Bangalore.
5. State Government letter No.FEE 56 FGL 2006, dated :12.11.2008.
6. Letter No. F©A/11.2/279/KAR/TL/3974, dated:13.03.2009 of Government of India, Ministry of Environment and Forests, Regional office(South Zone), Bangalore.

**Preamble:**

The Principal Chief Conservator of Forests, Bangalore vide his letter read at (1) above had submitted a proposal for diversion of 8.79 ha. of forest land in Koppa Forest Division for construction of 33 KV DC line from Muthinakoppa Substation to N.R.Pura Substation and N.R.Pura Substation to Koppa Substation in N.R.Pura Taluk, Chickmagalur District in favour of Executive Engineer (Elect) MESCOM Ltd., Chickmagalur subject to certain conditions. The details of the forest land required with Sy.Nos. details is as under:

| Name of the Forest | Name of the Village | Sy.No. | Area in ha. |
|---|---|---|---|
| Aramballi SF | Muthinakoppa | 74 | 0.08 |
| | Madabur | 57 | 4.21 |
| | Kadahinabylu | 20 | 0.60 |
| Maliandur SF | Gibbige | 109<br>37 | 1.74<br>0.31 |
| | Kadahinabylu | 112 | 0.21 |
| | Balekoppa MF | 37 | 0.52 |
| District Forest 1983-84 Plantation | Nagalapura | 179 | 0.37 |
| District Forest | Binthravalli | 188 | 0.75 |
| | **Total** | | **8.79** |

Accordingly, the proposal was recommended to Government of India, vide State Government letter dated: 20.07.2006 read at 2 above.

The Government of India, Ministry of Environment and Forests, Regional Office, South Zone, Bangalore vide their letter dated 25-05-2007 read at 3 above conveyed its approval (Stage-I) for diversion of 8.79 ha. of forest land subject to fulfillment of certain conditions and the same was communicated to the Principal Chief Conservator of Forests, Bangalore for compliance.

The Principal Chief Conservator of Forests, Bangalore vide his letter dated 04-09-2008 furnished the compliance report read at 4 above and the same has been sent to Government of India vide State Government letter dated: 12.11.2008 read at 5 above.

Government of India Ministry of Environment and Forests, Regional Office, South Zone, Bangalore vide their letter dated: 13.03.2009 read at 6 above has conveyed its approval (Stage-II) under Section 2 of Forest (Conservation) Act,1980 for diversion of 8.79 ha. of forest land in Koppa Forest Division for construction of 33 KV DC line from Muthinakoppa Substation to N.R.Pura Substation and N.R.Pura Substation to Koppa Substation in N.R.Pura Taluk, Chickmagalur District in favour of Executive Engineer (Elect) MESCOM Ltd., Chickmagalur subject to certain conditions.

The proposal has been examined in detail and hence the order.

**Government Oreder No. FEE 56 FGL 2006, Bangalore, Dated: 18th May 2009**

In the circumstances explained in the preamble above, Government is pleased to accord approval under section (2) of Forest (Conservation) Act 1980 for diversion of 8.79 ha. of forest land in Koppa Forest Division(Sy.Nos. mentioned in the preamble) for construction of 33 KV DC line from Muthinakoppa Substation to N.R.Pura Substation and N.R.Pura Substation to Koppa Substation in N.R.Pura Taluk, Chickmagalur District in favour of Executive Engineer (Elect) MESCOM Ltd., Chickmagalur subject to the following conditions:

1. The legal status of forest land shall remain unchanged.
2. Compensatory afforestation shall be raised over of equivalent identified non-forest land in Sy.No.7 of Hosur village, Koppa Taluk, at the cost of user agency. The State Government shall obtain prior permission of Central Government for change of location and schedule of Compensatory Afforestation, if any.
3. Non forest land for compensatory afforestation shall be notified by the State Government as RF/PF under Indian Forest Act, 1927 or the State Forest Act within a period of 6 months and Nodal Officer(FCA) shall report the compliance within 6 months.
4. The funds received from the user agency towards Compensatory Afforestation and Net Present Value under this project shall be transferred to Ad-hoc CAMPA in account number CA-1582 of Corporation Bank, Block-II, CGO Complex, Phase-I, Lodhi Road, New Delhi-110 003.
5. The additional amount of the NPV if any due as per the orders of the Hon`ble Supreme Court dated 28.03.2008 and 09.05.2008 in IA Nos.826 in 566 with related IA`s in Writ Petition(Civil) No.202/1995 shall be realised from the user agency and transferred to Ad-hoc CAMPA in account number CA-1578 of Corporation Bank, Block-II, CGO Complex, Phase-I, Lodhi Road, New Delhi-110 003 under intimation to Government of India.
6. The total forest area utilised for the project shall not exceed 8.79 ha. The forest area shall be utilised only for the purpose for which it is diverted. In case the land is not taken over by the user agency or the same is not used for the stipulated purpose within a period of two years, then the area will be resumed by the Forest Department under section 82 of Karnataka Forest Act 1963. The Conservator of Forests, Chickmagalore Circle, Chickmagalore is authorised to take necessary action in this regard. No residential buildings shall be permitted in the proposed area.
7. Only minimum number of trees shall be cut based on actual requirement for laying the KV line.
8. The lessee shall pay lease rent as fixed by the Government from time to time.
9. The lease is for a period of 30 years.

10. The Karnataka Forest Act, 1963 and Rules, 1969 will be applicable for any violation.
11. The user agency has to pay the Net Present Value (NPV) of forest land diverted under this proposal as per the orders of the Hon`ble Supreme Court dated 30.10.2002 and 01.08.2003 in IA 566 in Writ Petition No.202/1995 and as per guidelines issued by the Ministry vide letter No.5-1/1998-FC(pt-II), dated: 18.9.2003 and 22.9.2003 and State Government Order dated: 17.1.2004.
12. Trees shall be felled only when it becomes necessary and under strict supervision of State Forest Department.
13. The usr agency shall pay the cost of extraction of trees if available as estimated by the Department.
14. The user agency shall ensure that there should be no damage to the available Wildlife.
15. The user agency shall abide by all the conditions imposed upon by Government of India, Government of Karnataka and Principal Chief Conservator of Forests.
16. Any other conditions to be imposed by the Government of India/Government of Karnataka /Principal Chief Conservator of Forests will be abided by the lessee.

By Order and in the name of the Governor of Karnataka,

**H.M. MALLIKARJUANA SWAMY**

P.R. 1403

Under Secretary to Government,

Forest, Ecology and Environment Department.

**Sub:** Diversion of 0.112 ha. of forest land in Ft.Sy.No.87A of Venkatapur village and Ft. Sy.No.61 of Bilalkhand village for construction of the Water Treatment Plant for supply of water to Jali Gram Panhcyat, Bhatkal Taluk under Jal Nirmal Project.

**Read:**
1. Letter No.A5(2)GFL.CR.3/07-08 dated: 29/05/2007 and 05/11/2007 of the Principal Chief Conservator of Forests, Bangalore.
2. State Government letter No.FEE 70 FLL 2007, dated: 27.11.2007.
3. Letter No.4-KRB-382/2007-BAN/1410, dated: 10-12-2007 of Government of India, Ministry of Environment and Forests, Regional Office, South Zone, Bangalore.
4. Letter No.A5(2)GFL.CR.3/07-08 dated: 27/02/2009 of the Principal Chief Conservator of Forests, Bangalore.
5. State Government letter No.FEE 70 FLL 2007, dated: 24.04.2009.
6. Letter No.4-KRB-382/2007-BAN/4348, dated: 12-05-2009 of Government of India, Ministry of Environment and Forests, Regional Office, South Zone, Bangalore.

**Preamble:**

The Principal Chief Conservator of Forests, Bangalore vide his letter dated: 29/05/2007 and 05/11/2007 read at (1) above has submitted the proposal and revised proposal to obtain the approval of Government of India under Section 2 of the Forest (Conservation) Act, 1980 for diversion of 0.112 ha. of forest land in Ft.Sy.No.87A of Venkatapur village and Ft. Sy.No.61 of Bilalkhand village for construction of the Water Treatment Plant for supply of water to Jali Gram Panchyat, Bhatkal Taluk under Jal Nirmal Project in favour of Project Manager, ZP, PSU, Jal Nirmal Project, U.K.District, Karwar subject to certain conditions.

Accordingly, the proposal was recommended to Government of India vide State Government letter dated: 27.11.2007 read at (2) above.

The Government of India, Ministry of Environment and Forests, Regional office, Bangalore vide their letter dated: 10-12-2007 read at (3) above has given its in principle (Stage-I) approval subject to fulfillment of certain conditions and the same was communicated to the Principal Chief Conservator of Forests, Bangalore for compliance.

The Principal Chief Conservator of Forests, Bangalore vide his letter dated: 27.02.2009 read at (4) above furnished the compliance report and the same has been sent to Government of India vide State Government letter dated: 24-04-2009 read at 5 above.

Government of India, Ministry of Environment and Forests, Regional Office, South Zone, Bangalore vide their letter dated: 12.05.2009 read at (5) above conveyed its approval (Stage-II) under Section 2 of the Forest(Conservation)Act, 1980 for diversion of 0.112 ha. of forest land in Ft.Sy.No.87A of Venkatapur village and Ft. Sy.No.61 of Bilalkhand village for construction of the Water Treatment Plant for supply of water to Jali Gram Panchayat, Bhatkal Taluk under Jal Nirmal Project in favour of Project Manager, ZP, PSU, Jal Nirmal Project, U.K.District, Karwar subject to certain conditions.

The proposal has been examined in detail and hence the order.

**Government Oreder No. FEE 70 FLL 2007, Bangalore, Dated: 29th May 2009**

In the circumstances explained in the preamble above, Government are pleased to accord sanction under section (2) of Forest (Conservation) Act 1980 for diversion of 0.112 ha. of forest land in Ft.Sy.No.87A of Venkatapur village and Ft. Sy.No.61 of Bilalkhand village for construction of the Water Treatment Plant for supply of water to Jali Gram Panchayat, Bhatkal Taluk under Jal Nirmal Project in favour of Project Manager, ZP, PSU, Jal Nirmal Project, U.K.District, Karwar subject to the following conditions:

1. The legal status of forest land shall remain unchanged.
2. The funds received from the user agency towards NPV under this project shall be transferred to Ad-hoc CAMPA in account number CA 1582 of Corporation Bank, Block-II, CGO Complex, Phase-I, Lodhi Road, New Delhi-110 003.
3. The additional amount of the Net Present Value(NPV) of the diverted forest land if any, due as per the orders of the Hon`ble Supreme Court dated: 28.03.2008 and 09.05.2008 in IA Nos. 826 in 566 with related IA`s in Writ Petition(Civil) No.202/1995 shall be realised from the user agency and transferred to Ad-hoc CAMPA in account number CA-1582 of Corporation Bank, Block-II, CGO Complex, Phase-I, Lodhi Road, New Delhi-110 003 under intimation to Government of India.
4. The total forest area utilized for the project shall not exceed 0.112 ha. The forest area shall be used only for the purpose for which it is diverted. In case the land is not taken over by the user agency or the same is not used for the stipulated purpose within a period of two years then the area will be taken back by the Forest Department by the Conservator of Forests under section 82 of Karnataka Forest Act, 1963.
5. The user agency has to pay the lease rent as fixed by the Government at the time of sanction and any subsequent orders in this regard.
6. The lease is granted for 20 years.
7. The Karnataka Forest Act, 1963 and Rules, 1969 will be applicable for any violation.
8. The user agency has to pay the Net Present Value as per the Government Notification dated: 17.1.2004, @ Rs. 5.80 to Rs. 9.20 lakhs per ha. depending upon the quantity and density of the land.
9. Any other conditions to be imposed by the Government of India/Government of Karnataka /Principal Chief Conservator of Forests will be abided by the lessee.

By Order and in the name of the Governor of Karnataka,

**H.M. MALLIKARJUNASWAMY**

P.R. 1404

Under Secretary to Government,

Forest, Ecology and Environment Department.

## ಜಲಸಂಪನ್ಮೂಲ ಸಚಿವಾಲಯ

**ವಿಷಯ:** ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ನಿಡಶೇಷಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಬ್ಯಾಲಿಹಾಳ ಗ್ರಾಮದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ 03/03/09ರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ ಭೂಸ್ವಾಪ್ರ/2008–09/1734.

**ಪ್ರಸ್ತಾವನೆ:**

ಮೇಲೆ ಓದಲಾದ ಬಿಜಾಪುರ ಸಣ್ಣ ನೀರಾವರಿ ಉತ್ತರ ವಲಯದ ಮುಖ್ಯ ಇಂಜಿನಿಯರ್ ರವರ ಪತ್ರದಲ್ಲಿ ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ನಿಡಶೇಷಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಬ್ಯಾಲಿಹಾಳ ಗ್ರಾಮದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ.ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ: 31/10/1996.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ: 09/06/1999.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನಾಧಿಕಾರಿಗಳ ಪರಿಹಾರ ಧನದ ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಕೊಪ್ಪಳದ ಸಿವಿಲ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ಭೂಸ್ವಾಧೀನ ಪ್ರಕರಣ ದಾಖಲಿಸಿದ್ದು, ಈ ಪ್ರಕರಣದಲ್ಲಿ ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದೆ. ಸಿವಿಲ್ ನ್ಯಾಯಾಲಯದ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಾನೂನು ಇಲಾಖೆಯು ಪತ್ರ ಸಂಖ್ಯೆ:ಲಾ 3190 ಎಲ್ಎಸ್‌ಪಿ 2005, ದಿನಾಂಕ 27/02/2006ರಲ್ಲಿ ಅಭಿಪ್ರಾಯ ನೀಡಿದೆ.

ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ:

| ಕ್ರ. ಸಂ | ಎಲ್ಎಸಿ ಸಂಖ್ಯೆ | ಬ್ಯಾಲಿಹಾಳ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ. | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|
| 1 | 79/02 | 7/1ಎ | 8–35 | 2001037 |
| 2 | 78/02 | 11/2ಎ | 3–28 | 834527 |
| 3 | 80/02 | 11/2ಇ | 0–25 | 141383 |
| | ಒಟ್ಟು | | | 2976947 |

ಪರಿಹಾರ ಧನದ ಮೊತ್ತದಲ್ಲಿ ನ್ಯಾಯಾಲಯದ ವೆಚ್ಚ ಸಹ ಸೇರಿದೆ.

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸನೀಇ 47 ಭೂಸ್ವಾಪ್ರ 2009, ಬೆಂಗಳೂರು, ದಿನಾಂಕ: 26ನೇ ಜೂನ್ 2009**

ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ನಿಡಶೇಷಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಬ್ಯಾಲಿಹಾಳ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣದಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.29,76,947–00ಗಳನ್ನು (ಇಪ್ಪತ್ತೊಂಭತ್ತು ಲಕ್ಷದ ಎಪ್ಪತ್ತಾರು ಸಾವಿರದ ಒಂಭೈನೂರ ನಾಲ್ವತ್ತೇಳು ರೂಪಾಯಿಗಳು ಮಾತ್ರ) ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

ಈ ವೆಚ್ಚವನ್ನು 2009–10ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ 4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ಭರಿಸಿಕೊಳ್ಳತಕ್ಕದ್ದು.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಕೂಡಲೇ ಸಂಬಂಧಿಸಿದ ಸಣ್ಣ ನೀರಾವರಿ ಅಧಿಕಾರಿಗಳು ವರ್ಗಾವಣೆ ಬಗ್ಗೆ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2008, ದಿನಾಂಕ:16/05/2008ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರ ದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1413

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

**ವಿಷಯ:** ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ನಿಡಶೇಷಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಮದಲಗಟ್ಟಿ ಗ್ರಾಮದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ 03/03/09ರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ ಭೂಸ್ವಾಪ್ರ/2008–09/1732.

**ಪ್ರಸ್ತಾವನೆ:**

ಮೇಲೆ ಓದಲಾದ ಬಿಜಾಪುರ ಸಣ್ಣ ನೀರಾವರಿ ಉತ್ತರ ವಲಯದ ಮುಖ್ಯ ಇಂಜಿನಿಯರ್ ರವರ ಪತ್ರದಲ್ಲಿ ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ನಿಡಶೇಷಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಮದಲಗಟ್ಟಿ ಗ್ರಾಮದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 03/10/1996.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 09/06/1999.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನಾಧಿಕಾರಿಗಳ ಪರಿಹಾರ ಧನದ ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಕೊಪ್ಪಳದ ಸಿವಿಲ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ಭೂಸ್ವಾಧೀನ ಪ್ರಕರಣ ದಾಖಲಿಸಿದ್ದು, ಈ ಪ್ರಕರಣದಲ್ಲಿ ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದೆ. ಸಿವಿಲ್ ನ್ಯಾಯಾಲಯದ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಾನೂನು ಇಲಾಖೆಯ ಪತ್ರ ಸಂಖ್ಯೆ: ಲಾ 2384 ಎಲ್ಎಸ್‌ಪಿ 2005, ದಿನಾಂಕ 23/02/2006ರಲ್ಲಿ ಅಭಿಪ್ರಾಯ ನೀಡಿದೆ.

ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ:

| ಕ್ರ. ಸಂ | ಎಲ್ಎಸಿ ಸಂಖ್ಯೆ | ಮದಲಗಟ್ಟಿ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ. | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|
| 1 | 21/01 | 8 | 11–04 | 2370984 |
| 2 | 20/01 | 7/2ಬಿ | 5–00 | 1068286 |
| 3 | 15/01 | 5/2 | 6–13 | 1351249 |
| 4 | 14/01 | 5/1ಎ | 6–34 | 1463365 |
| | ಒಟ್ಟು | | | 6253884 |

ಪರಿಹಾರ ಧನದ ಮೊತ್ತದಲ್ಲಿ ನ್ಯಾಯಾಲಯದ ವೆಚ್ಚ ಸಹ ಸೇರಿದೆ.

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸನೀಇ 49 ಭೂಸ್ವಾಪ್ರ 2009, ಬೆಂಗಳೂರು, ದಿನಾಂಕ: 26ನೇ ಜೂನ್ 2009**

ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ನಿಡಶೇಷಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಮದಲಗಟ್ಟಿ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣದಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.62,53,884–00ಗಳನ್ನು (ಅರವತ್ತೆರಡು ಲಕ್ಷದ ಐವತ್ತಮೂರು ಸಾವಿರದ ಎಂಟು ನೂರ ಎಂಭತನಾಲ್ಕು ರೂಪಾಯಿಗಳು ಮಾತ್ರ) ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

ಈ ವೆಚ್ಚವನ್ನು 2009–10ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ 4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ಭರಿಸಿಕೊಳ್ಳತಕ್ಕದ್ದು.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಕೂಡಲೇ ಸಂಬಂಧಿಸಿದ ಸಣ್ಣ ನೀರಾವರಿ ಅಧಿಕಾರಿಗಳು ವರ್ಗಾವಣೆ ಬಗ್ಗೆ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2008, ದಿನಾಂಕ:16/05/2008ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರ ದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1414

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

**ವಿಷಯ:** ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ನಿಡಶೇಷಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿ ಕೊಳ್ಳಲಾದ ಬೆಂಚಮಟ್ಟಿ ಗ್ರಾಮದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ 03/03/09ರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ ಭೂಸ್ವಾಪ್ರ/2008–09/1735.

**ಪ್ರಸ್ತಾವನೆ:**

ಮೇಲೆ ಓದಲಾದ ಬಿಜಾಪುರ ಸಣ್ಣ ನೀರಾವರಿ ಉತ್ತರ ವಲಯದ ಮುಖ್ಯ ಇಂಜಿನಿಯರ್ ರವರ ಪತ್ರದಲ್ಲಿ ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ನಿಡಶೇಷಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಬೆಂಚಮಟ್ಟಿ ಗ್ರಾಮದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ.ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ: 03/10/1996.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ: 18/07/1999.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನಾಧಿಕಾರಿಗಳ ಪರಿಹಾರ ಧನದ ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಕೊಪ್ಪಳದ ಸಿವಿಲ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ಭೂಸ್ವಾಧೀನ ಪ್ರಕರಣಗಳನ್ನು ದಾಖಲಿಸಿದ್ದು, ಈ ಪ್ರಕರಣಗಳಲ್ಲಿ ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದೆ. ಸಿವಿಲ್ ನ್ಯಾಯಾಲಯದ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಾನೂನು ಇಲಾಖೆಯು ಪತ್ರ ಸಂಖ್ಯೆ:ಲಾ 2521 ಎಲ್ಎಸ್‌ಪಿ 2005, ದಿನಾಂಕ: 31/01/2006ರಲ್ಲಿ ಅಭಿಪ್ರಾಯ ನೀಡಿದೆ.

ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ:

| ಕ್ರ. ಸಂ | ಎಲ್ಎಸಿ ಸಂಖ್ಯೆ | ಬೆಂಚಮಟ್ಟಿ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ. | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|
| 1 | 411/2000 | 12/3ಎ | 3–29 | 1033887 |
| 2 | 406/2000 | 11/4 | 1–32 | 499855 |
| 3 | 408/2000 | 11/7 | 0–13 | 90661 |
| 4 | 409/2000 | 12/1<br>12/2<br>14/1–4<br>15/1/2 | 0–12<br>6–38<br>0–02<br>2–00 | 2580499 |
| 5 | 413/2000 | 13/5 | 0–20 | 139210 |
| 6 | 414/2000 | 13/6<br>13/7 | 1–16<br>1–00 | 666306 |
| 7 | 418/2000 | 13/1 | 0–24 | 166952 |
| 8 | 422/2000 | 15/2ಎ | 1–31 | 492919 |
| | | | ಒಟ್ಟು | **5670289** |

ಪರಿಹಾರ ಧನದ ಮೊತ್ತದಲ್ಲಿ ನ್ಯಾಯಾಲಯದ ವೆಚ್ಚ ಸಹ ಸೇರಿದೆ.

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸನೀಇ 52 ಭೂಸ್ವಾಪ್ರ 2009, ಬೆಂಗಳೂರು, ದಿನಾಂಕ: 26ನೇ ಜೂನ್ 2009**

ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ನಿಡಶೇಷಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಬೆಂಚಮಟ್ಟಿ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣದಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.56,70,289–00ಗಳನ್ನು (ಐವತ್ತಾರು ಲಕ್ಷದ ಎಪ್ಪತ್ತು ಸಾವಿರದ ಇನ್ನೂರ ಎಂಭತ್ತೊಂಭತ್ತು ರೂಪಾಯಿಗಳು ಮಾತ್ರ) ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

ಈ ವೆಚ್ಚವನ್ನು 2009–10ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ 4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ಭರಿಸಿಕೊಳ್ಳತಕ್ಕದ್ದು.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಕೂಡಲೇ ಸಂಬಂಧಿಸಿದ ಸಣ್ಣ ನೀರಾವರಿ ಅಧಿಕಾರಿಗಳು ವರ್ಗಾವಣೆ ಬಗ್ಗೆ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2008, ದಿನಾಂಕ:16/05/2008ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರ ದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1415 **ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

**ವಿಷಯ:** ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ಪುರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ 06/05/09ರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/ 2008–09/2773.

**ಪ್ರಸ್ತಾವನೆ:**

ಮೇಲೆ ಓದಲಾದ ಬಿಜಾಪುರ ಸಣ್ಣ ನೀರಾವರಿ ಉತ್ತರ ವಲಯದ ಮುಖ್ಯ ಇಂಜಿನಿಯರ್ ರವರ ಪತ್ರದಲ್ಲಿ ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ಪುರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಉದ್ಯಾಳ ಮತ್ತು ಯತ್ನಟ್ಟಿ ಗ್ರಾಮಗಳ ಜಮೀನುಗಳಿಗೆ ಕೊಪ್ಪಳದ ಸಿವಿಲ್ ನ್ಯಾಯಾಲಯವು (ಹಿರಿಯ ಶ್ರೇಣಿ) ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 14/02/02
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 29/07/05.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನಾಧಿಕಾರಿಗಳ ಪರಿಹಾರ ಧನದ ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಕೊಪ್ಪಳದ ಸಿವಿಲ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ಭೂಸ್ವಾಧೀನ ಪ್ರಕರಣಗಳನ್ನು ದಾಖಲಿಸಿದ್ದು, ಈ ಪ್ರಕರಣದಲ್ಲಿ ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದೆ. ಸಿವಿಲ್ ನ್ಯಾಯಾಲಯದ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಕೋಶವು ಪತ್ರ ಸಂಖ್ಯೆ:ಆರ್‌ಡಿ 312 ಎಲ್‌ಸಿಜಿ 2008 ಹಾಗೂ ಆರ್‌ಡಿ 316 ಎಲ್‌ಸಿಜಿ 2008, ದಿನಾಂಕ 16/02/09ರಲ್ಲಿ ಅಭಿಪ್ರಾಯ ನೀಡಿದೆ.

ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ:

| ಕ್ರ. ಸಂ | ಎಲ್‌ಎಸಿ ಸಂಖ್ಯೆ | ಸ.ನಂ. | ಗ್ರಾಮ | ವಿಸ್ತೀರ್ಣ ಎ–ಗುಂ. | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|---|
| 1 | 01/07 | 81 | ಉದ್ಯಾಳ | 0–32 | 267066 |
| 2 | 03/07 | 80/ಬಿ | ಉದ್ಯಾಳ | 0–10 | 83677 |
| 3 | 04/07 | 101/ಸಿ | ಯತ್ನಟ್ಟಿ | 0–08 | 67195 |
| 4 | 05/07 | 101/ಡಿ | ಯತ್ನಟ್ಟಿ | 0–16 | 134093 |
| 5 | 08/07 | 80/ಡಿ | ಉದ್ಯಾಳ | 0–30 | 250391 |
| 6 | 09/07 | 80/ಎ | ಉದ್ಯಾಳ | 0–10 | 83667 |
| 7 | 10/07 | 80 | ಉದ್ಯಾಳ | 0–10 | 83667 |
| 8 | 13/07 | 64/ಎ | ಉದ್ಯಾಳ | 0–20 | 167542 |
| 9 | 14/07 | 101/ಬಿ | ಯತ್ನಟ್ಟಿ | 0–16 | 134093 |
| 10 | 35/08 | 72/ಅ, 72/ಆ | ಯತ್ನಟ್ಟಿ | 1–34 | 619095 |
| | ಒಟ್ಟು | | | | **1890486** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 67 ಭೂಸ್ವಾಪ್ರ 2009, ಬೆಂಗಳೂರು, ದಿನಾಂಕ 26ನೇ ಜೂನ್ 2009.**

ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ಪುರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಮೇಲ್ಕಂಡ ಗ್ರಾಮಗಳ ಸ.ನಂ.ಗಳ ಜಮೀನುಗಳಿಗೆ ಕೊಪ್ಪಳದ ಸಿವಿಲ್ ನ್ಯಾಯಾಲಯವು (ಹಿರಿಯ ಶ್ರೇಣಿ) ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.18,90,486–00ಗಳನ್ನು (ಹದಿನೆಂಟು ಲಕ್ಷದ ತೊಂಭತ್ತು ಸಾವಿರದ ನಾನೂರ ಎಂಭತ್ತಾರು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ.

ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

ಈ ವೆಚ್ಚವನ್ನು 2009–10ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ 4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ಭರಿಸಿಕೊಳ್ಳತಕ್ಕದ್ದು.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಕೂಡಲೇ ಸಂಬಂಧಿಸಿದ ಸಣ್ಣ ನೀರಾವರಿ ಅಧಿಕಾರಿಗಳು ವರ್ಗಾವಣೆ ಬಗ್ಗೆ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2008, ದಿನಾಂಕ 16/05/2008ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರ ದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1416

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

**ವಿಷಯ:** ಗುಲ್ಬರ್ಗಾ ಜಿಲ್ಲೆ, ಶಹಾಪುರ ತಾಲ್ಲೂಕು ಕರದಳ್ಳಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ 04/02/09ರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/ 2008–09/709.

**ಪ್ರಸ್ತಾವನೆ:**

ಮೇಲೆ ಓದಲಾದ ಬಿಜಾಪುರ ಸಣ್ಣ ನೀರಾವರಿ ಉತ್ತರ ವಲಯದ ಮುಖ್ಯ ಇಂಜಿನಿಯರ್ ರವರ ಪತ್ರದಲ್ಲಿ ಗುಲ್ಬರ್ಗಾ ಜಿಲ್ಲೆ, ಶಹಾಪುರ ತಾಲ್ಲೂಕು ಕರದಳ್ಳಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ರೂ.2,55,205–00ಗಳ ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 24/04/97
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 20/05/98

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನಾಧಿಕಾರಿಗಳ ಪರಿಹಾರ ಧನದ ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಶೋರಾಪೂರ ಸಿವಿಲ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ಭೂಸ್ವಾಧೀನ ಪ್ರಕರಣವನ್ನು ದಾಖಲಿಸಿದ್ದು, ಈ ಪ್ರಕರಣದಲ್ಲಿ ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದೆ.

ಸಿವಿಲ್ ನ್ಯಾಯಾಲಯದ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯು ಪತ್ರ ಸಂಖ್ಯೆ:ಆರ್‌ಡಿ 624 ಎಲ್‌ಸಿಜಿ 2009, ದಿನಾಂಕ 21/05/09ರಲ್ಲಿ ಅಭಿಪ್ರಾಯ ನೀಡಿದೆ.

ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ:

| ಕ್ರ. ಸಂ | ಎಲ್‌ಎಸಿ ಸಂಖ್ಯೆ | ಕರದಳ್ಳಿ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ. | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|
| 1 | 159/04 | 179/ಎ | 2–21 | 2,55,205–00 |

ಪರಿಹಾರ ಧನದ ಮೊತ್ತದಲ್ಲಿ ನ್ಯಾಯಾಲಯದ ವೆಚ್ಚ ಸಹ ಸೇರಿದೆ.

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 27 ಭೂಸ್ವಾಪ್ರ 2009, ಬೆಂಗಳೂರು, ದಿನಾಂಕ 23ನೇ ಜೂನ್ 2009.**

ಗುಲ್ಬರ್ಗಾ ಜಿಲ್ಲೆ, ಶಹಾಪುರ ತಾಲ್ಲೂಕು ಕರದಳ್ಳಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಕರದಳ್ಳಿ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ನ ಜಮೀನಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.2,55,205–00ಗಳನ್ನು (ಎರಡು ಲಕ್ಷದ ಐವತ್ತೈದು ಸಾವಿರದ ಇನ್ನೂರ ಐದು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

ಈ ವೆಚ್ಚವನ್ನು 2009–10ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ 4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ಭರಿಸಿಕೊಳ್ಳತಕ್ಕದ್ದು.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಕೂಡಲೇ ಸಂಬಂಧಿಸಿದ ಸಣ್ಣ ನೀರಾವರಿ ಅಧಿಕಾರಿಗಳು ವರ್ಗಾವಣೆ ಬಗ್ಗೆ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2008, ದಿನಾಂಕ 16/05/2008ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರ ದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1417

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**ವಿಷಯ:** ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ನಿಡಶೇಷಿ ಗ್ರಾಮದ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ 03/03/09ರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ ಭೂಸ್ವಾಪ್ರ/2008–09/1733.

**ಪ್ರಸ್ತಾವನೆ:**

ಮೇಲೆ ಓದಲಾದ ಬಿಜಾಪುರ ಸಣ್ಣ ನೀರಾವರಿ ಉತ್ತರ ವಲಯದ ಮುಖ್ಯ ಇಂಜಿನಿಯರ್ ರವರ ಪತ್ರದಲ್ಲಿ ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ನಿಡಶೇಷಿ ಗ್ರಾಮದ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಸದರಿ ಗ್ರಾಮದ ಸರ್ವೆ ನಂಬರ್‌ಗಳ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 17/10/1996
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 16/04/1999

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನಾಧಿಕಾರಿಗಳ ಪರಿಹಾರ ಧನದ ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಕೊಪ್ಪಳದ ಸಿವಿಲ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ಭೂಸ್ವಾಧೀನ ಪ್ರಕರಣಗಳನ್ನು ದಾಖಲಿಸಿದ್ದು, ಈ ಪ್ರಕರಣಗಳಲ್ಲಿ ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದೆ. ಸಿವಿಲ್ ನ್ಯಾಯಾಲಯದ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಾನೂನು ಇಲಾಖೆಯು ಪತ್ರ ಸಂಖ್ಯೆ:ಲಾ 2945 ಎಲ್‌ಎಸ್‌ಪಿ 2005, ದಿನಾಂಕ 23/02/06ರಲ್ಲಿ ಅಭಿಪ್ರಾಯ ನೀಡಿದೆ.

ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ:

| ಕ್ರ. ಸಂ | ಎಲ್‌ಎಸಿ ಸಂಖ್ಯೆ | ಸ.ನಂ. | ವಿಸ್ತೀರ್ಣ ಎ–ಗುಂ. | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|
| 1 | 443/00 | 25/ಬಿ | 1–05 | 271442 |
| 2 | 439/00 | 26 | 1–16 | 337673 |
| 3 | 440/00 | 27/1 | 0–20 | 120919 |
| 4 | 445/00 | 18 | 1–00 | 241338 |
| | | | 4–25 | 1114375 |
| | ಒಟ್ಟು | | | **2085747** |

ಪರಿಹಾರ ಧನದ ಮೊತ್ತದಲ್ಲಿ ನ್ಯಾಯಾಲಯದ ವೆಚ್ಚ ಸಹ ಸೇರಿದೆ.

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸನೀಇ 50 ಭೂಸ್ವಾಪ್ರ 2009, ಬೆಂಗಳೂರು, ದಿನಾಂಕ: 26ನೇ ಜೂನ್ 2009.**

ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ನಿಡಶೇಷಿ ಗ್ರಾಮದ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ನಿಡಶೇಷಿ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.20,85,747–00ಗಳನ್ನು (ಇಪ್ಪತ್ತು ಲಕ್ಷದ ಎಂಭತ್ತೈದು ಸಾವಿರದ ಏಳು ನೂರ ನಾಲ್ವತ್ತೇಳು ರೂಪಾಯಿಗಳು ಮಾತ್ರ) ಪಾವತಿಸಲು ಅನುಮೋದನೆ ನೀಡಿದೆ. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

ಈ ವೆಚ್ಚವನ್ನು 2009–10ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ 4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ಭರಿಸಿಕೊಳ್ಳತಕ್ಕದ್ದು.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಕೂಡಲೇ ಸಂಬಂಧಿಸಿದ ಸಣ್ಣ ನೀರಾವರಿ ಅಧಿಕಾರಿಗಳು ವರ್ಗಾವಣೆ ಬಗ್ಗೆ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2008, ದಿನಾಂಕ 16/05/2008ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರ ದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1418 **ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ).

**ವಿಷಯ:** ಗುಲ್ಬರ್ಗಾ ಜಿಲ್ಲೆ, ಚಿಂಚೋಳಿ ತಾಲ್ಲೂಕು ಕೂಡ್ಲಿ ಅಲ್ಲಾಪುರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಧನ ಪಾವತಿಸುವ ಕುರಿತು.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ: 05/12/2008ರ ಪತ್ರ ಸಂಖ್ಯೆ: ಮುಇಂ/ಸನೀ/(ಉ)ವ/ ಬಿಜಾ/ಭೂಸ್ವಾಪ್ರ/2008–09/4445.

**ಪ್ರಸ್ತಾವನೆ:–**

ಮೇಲೆ ಓದಲಾದ ಬಿಜಾಪುರ ಸಣ್ಣ ನೀರಾವರಿ ಉತ್ತರ ವಲಯದ ಮುಖ್ಯ ಇಂಜಿನಿಯರ್ ರವರ ಪತ್ರದಲ್ಲಿ ಗುಲ್ಬರ್ಗಾ ಜಿಲ್ಲೆ ಚಿಂಚೋಳಿ ತಾಲ್ಲೂಕು ಕೂಡ್ಲಿ ಅಲ್ಲಾಪುರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯವು ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರ ಧನ ಪಾವತಿಸಲು ರೂ. 4,96,015/–ಗಳ ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತ್ತಿರುತ್ತದೆ:

ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ: 04/05/1995.

ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ: 25/06/1997.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನಾಧಿಕಾರಿಗಳ ಪರಿಹಾರ ಧನದ ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಸೇಡಂ ಸಿವಿಲ್ ನ್ಯಾಯಾಲಯದಲ್ಲಿ ಪ್ರಕರಣ ದಾಖಲಿಸಿದ್ದು, ಈ ಪ್ರಕರಣದಲ್ಲಿ ಸಿವಿಲ್ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀಪು ನೀಡಿದೆ. ಭೂಮಾಲೀಕರು ಸಿವಿಲ್ ನ್ಯಾಯಾಲಯವು ಹೆಚ್ಚಿಸಿದ್ದ ಪರಿಹಾರ ಧನಕ್ಕಿಂತ ಇನ್ನೂ ಹೆಚ್ಚಿನ ಪರಿಹಾರ ಧನಕ್ಕಾಗಿ ಉಚ್ಚ ನ್ಯಾಯಾಲಯದಲ್ಲಿ ಎಂ.ಎಫ್.ಎ ಪ್ರಕರಣಗಳನ್ನು ದಾಖಲಿಸಿರುತ್ತಾರೆ. ಉಚ್ಚ ನ್ಯಾಯಾಲಯವು ಸಿವಿಲ್ ನ್ಯಾಯಾಲಯವು ಹೆಚ್ಚಿಸಿದ ಪರಿಹಾರ ಧನಕ್ಕಿಂತ ಇನ್ನು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿರುತ್ತದೆ.

ಉಚ್ಚ ನ್ಯಾಯಾಲಯದ ತೀರ್ಪಿನ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಾನೂನು ಇಲಾಖೆಯ ಪತ್ರ ಸಂಖ್ಯೆ: 1) ಲಾ 2374 ಎಲ್.ಎಸ್.ಪಿ 2007 ದಿನಾಂಕ: 02/06/2008 2) ಲಾ 1009 ಎಲ್.ಎಸ್.ಪಿ 2007 ದಿನಾಂಕ: 17/10/2008 ಹಾಗೂ 3) ಲಾ 1016 ಎಲ್.ಎಸ್.ಪಿ 2007 ದಿನಾಂಕ: 13/10/2008ರಲ್ಲಿ ಅಭಿಪ್ರಾಯ ನೀಡಿದೆ.

ಉಚ್ಚ ನ್ಯಾಯಾಲಯವು ಹೆಚ್ಚಿನ ಪರಿಹಾರ ಧನಕ್ಕೆ ತೀರ್ಪು ನೀಡಿರುವ ಪ್ರಕರಣದ ವಿವರ ಕೆಳಕಂಡಂತಿದೆ:

| ಕ್ರ. ಸಂ. | ಎಲ್ಎಸಿ ಪ್ರಕರಣ ಸಂಖ್ಯೆ | ಎಂ.ಎಫ್.ಎ ಸಂಖ್ಯೆ | ಕೂಡ್ಲಿ ಅಲ್ಲಾಪುರ ಗ್ರಾಮದ ಸ. ನಂ | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|---|
| 01 | 1/02 | 6583/05 | 43 | 2–08 | 222709 |
| 02 | 279/02 | 1791/05 | 65/1 | 1–14 | 133295 |
| 03 | 279/02 | 6584/05 | 65/2 | 1–14 | 140011 |
| **ಒಟ್ಟು** | | | | | **496015** |

ಪರಿಹಾರ ಧನದ ಮೊತ್ತದಲ್ಲಿ ನ್ಯಾಯಾಲಯದ ವೆಚ್ಚ ಸಹ ಸೇರಿದೆ.

ಪ್ರಸ್ತಾವನೆಯನ್ನು ಕೂಲಂಕುಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಸನೀಇ 1 ಭೂಸ್ವಾಪ್ರ 2009, ಬೆಂಗಳೂರು, ದಿನಾಂಕ: 27ನೇ ಜೂನ್ 2009**

ಗುಲ್ಬರ್ಗಾ ಜಿಲ್ಲೆ, ಚಿಂಚೋಳಿ ತಾಲ್ಲೂಕು ಕೂಡ್ಲಿ ಅಲ್ಲಾಪುರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಕೂಡ್ಲಿ ಅಲ್ಲಾಪುರ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ನ ಜಮೀನುಗಳಿಗೆ ನ್ಯಾಯಾಲಯವು ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕ ಹಾಕಿದ ಪರಿಹಾರ ಧನ ಮೊತ್ತ ರೂ. 4,96,015/–ಗಳನ್ನು (ನಾಲ್ಕು ಲಕ್ಷದ ತೊಂಭತ್ತಾರು ಸಾವಿರದ ಹದಿನೈದು ರೂಪಾಯಿಗಳು ಮಾತ್ರ) ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಡೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

ಈ ವೆಚ್ಚವನ್ನು 2009–10ನೇ ಸಾಲಿನ ಆಯವ್ಯಯದ ಲೆಕ್ಕ ಶೀರ್ಷಿಕೆ 4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳ ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ಭರಿಸಿಕೊಳ್ಳತಕ್ಕದ್ದು.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಕೂಡಲೇ ಸಂಬಂಧಿಸಿದ ಸಣ್ಣ ನೀರಾವರಿ ಅಧಿಕಾರಿಗಳು ವರ್ಗಾವಣೆ ಬಗ್ಗೆ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ: ಎಫ್‌ಡಿ 01 ಟಿಎಫ್‌ಪಿ 2008 ದಿನಾಂಕ: 16/05/2008ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

ಪಿ.ಆರ್. 1419

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

**ಒಳಾಡಳಿತ ಸಚಿವಾಲಯ**

**ವಿಷಯ:** ಶ್ರೀ ಎಸ್.ಆರ್. ಪಾಟೀಲ್, ಪಿ.ಐ., ಬಾಗಲಕೋಟೆ ಜಿಲ್ಲೆ, ಇವರು ಸರ್ಕಾರಕ್ಕೆ ಸಲ್ಲಿಸಿರುವ ಪರಿಷ್ಕರಣ ಮೇಲ್ಮನವಿ ಅರ್ಜಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:** 1) ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಬೆಳಗಾವಿ, ಇವರ ಆದೇಶ ಸಂಖ್ಯೆ:ಸಿಬ್ಬಂದಿ 2ಎ/ಪಿಆರ್/06/ 2007 [ಅ.ಪು.ಸಂ:537/07] ದಿನಾಂಕ: 15–05–07

2) ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಉತ್ತರವಲಯ, ಬೆಳಗಾವಿ, ಇವರ ಆದೇಶ ಸಂಖ್ಯೆ:ಅಪೀಲು 165/ಉವ/2007 ದಿನಾಂಕ: 04–01–08

3) ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ:06–08–09

4) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಸಿಬಿ(8)79/2008–09 ದಿ:19–03–2009

**ಪ್ರಸ್ತಾವನೆ:–**

ಶ್ರೀ ಎಸ್.ಆರ್. ಪಾಟೀಲ್, ಪಿ.ಐ., ಇವರು ಕ್ಯಾಂಪ್ ಪೊಲೀಸ್ ಠಾಣೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ, ಇವರ ವಿರುದ್ಧ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯದಲ್ಲಿ ಘೋರ ನಿಷ್ಕಾಳಜಿತನ ಹಾಗೂ ಬೇಜವಾಬ್ದಾರಿತನವನ್ನು ಪ್ರದರ್ಶಿಸಿದ ಕಾರಣದ ಮೇಲೆ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿಗಳು) ನಿಯಮಾವಳಿ 1965ರ ನಿಯಮ 7 ರಡಿ ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿತ್ತು.

**ದೋಷರೋಪಣೆ:–**

> "ಆಪಾದಿತ ಪೊಲೀಸ್ ಅಧಿಕಾರಿಯಾದ ನೀವು ದಿ:04–10–2006 ರಂದು ಕರ್ನಾಟಕ ರಾಜ್ಯ ಬೆಳಗಾವಿಯ ಕರ್ನಾಟಕ ರಕ್ಷಣಾ ವೇದಿಕೆಯವರು ಹಾಗೂ ಬೆಳಗಾವಿ ಕನ್ನಡ ಸಂಘಟನೆಗಳು ಗಡಿ ವಿವಾದದ ಕುರಿತು ಕೇಂದ್ರ ಸರ್ಕಾರದ ನೀತಿ ವಿರುದ್ಧ ಕರ್ನಾಟಕ ಬಂದ್ ಆಚರಣೆಯ ಸಮಯದಲ್ಲಿ ಕನ್ನಡಪರ ಸಂಘಟನೆ ಜನರು ಬಂದು ಮರಾಠಿ ಭಾಷಿಕರ ಅಂಗಡಿಗಳನ್ನು ಬಂದ್ ಮಾಡಿಸುವಾಗ ಮರಾಠಿ ಜನರಿಗೂ ಹಾಗೂ ಕನ್ನಡಪರ ಜನ ರೊಂದಿಗೆ ವಾದ ವಿವಾದ ಆಗಿ ಕಾನೂನು ಮತ್ತು ಸುವ್ಯವಸ್ಥೆ ಭಂಗ ತರುವಂತಹ ಸಂದರ್ಭದಲ್ಲಿ ಎಪಿಎಂಸಿ ಠಾಣೆ, ಪಿ.ಎಸ್.ಐ. ಶ್ರೀ.ಜಾವೀದ್ ಎಸ್ ಮುಶಾಪುರಿ ರವರು ಮೊಬೈಲ್ ಮುಖಾಂತರ ಸಂಪರ್ಕಿಸಿ ನಿಮಗೆ ಬರಲು ತಿಳಿಸಿದಾಗ ನೀವು ಕೂಡಲೇ ಘಟನಾ ಸ್ಥಳಕ್ಕೆ ಬಂದು ಮುಂಜಾಗ್ರತಾ ಕ್ರಮ ಕೈಗೊಂಡು ಕಾನೂನು ಮತ್ತು ಸುವ್ಯವಸ್ಥೆ ಕಾಪಾಡುವಲ್ಲಿ ವಿಫಲರಾಗಿದ್ದಲ್ಲದೆ, ಎ.ಪಿ.ಎಂ.ಸಿ. ಗುನ್ನ ನಂ:111/06 ನೇದ್ದರಲ್ಲಿ ದಸ್ತಗೀರಾದ ಆರೋಪಿತರಾದ 1) ವಿನಾಯಕ ಹೊನಗೇಕರ 2) ಉದಯ ಸಿದ್ದನ್ನವರ ಇವರನ್ನು ಠಾಣೆಯಿಂದ ಕಳುಹಿಸಿಕೊಟ್ಟು ನಿಮ್ಮ ಕರ್ತವ್ಯದಲ್ಲಿ ಘೋರ ನಿಷ್ಕಾಳಜಿತನ ಹಾಗೂ ಬೇಜವಾಬ್ದಾರಿತನವನ್ನು ಪ್ರದರ್ಶಿಸಿರುವಿರಿ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಬೆಳಗಾವಿ, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 15–05–07ರ ಆದೇಶದಲ್ಲಿ "ಅರ್ಜಿದಾರರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ತದನಂತರದ ವಾರ್ಷಿಕ ವೇತನ ಬಡ್ತಿಗಳ ಮೇಲೆ ಪರಿಣಾಮ ಬೀರದಂತೆ ಎರಡು ವರ್ಷಕಾಲ ಮುಂದೂಡಲಾದ ದಂಡನೆ ವಿಧಿಸಿರುತ್ತಾರೆ."

ಈ ಆದೇಶದ ವಿರುದ್ದ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಉತ್ತರವಲಯ, ಬೆಳಗಾವಿ, ಇವರು ಶಿಸ್ತು ಪ್ರಾಧಿಕಾರದ ದಂಡನೆಯು ಆರೋಪಕ್ಕೆ ಅನುಗುಣವಾಗಿಲ್ಲವೆಂದು ಅಭಿಪ್ರಾಯಪಟ್ಟು ಇವರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ಮುಂದಿನ ವಾರ್ಷಿಕ ವೇತನ ಬಡ್ತಿಗಳ ಮೇಲೆ ಪರಿಣಾಮ ಬೀರದಂತೆ ಆರು ತಿಂಗಳ ಕಾಲ ಮೇಲೆ ಕ್ರಮ ಸಂಖ್ಯೆ:(2)ರಲ್ಲಿ ಓದಲಾದ ದಿನಾಂಕ:04–01–08ರ ಆದೇಶದಲ್ಲಿ ಶಿಸ್ತುಪ್ರಾಧಿಕಾರದ ದಂಡನಾದೇಶವನ್ನು ಮಾರ್ಪಡಿಸಿದ್ದಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನೂ, ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಪರಿಷ್ಕರಣ ಮೇಲ್ಮನವಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಅತೀವ ನಿರ್ಲಕ್ಷತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ, ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಒಇ 312 ಪೊಸಿಅ 2008 ಬೆಂಗಳೂರು, ದಿನಾಂಕ: 29ನೇ ಮೇ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಎಸ್.ಆರ್. ಪಾಟೀಲ್, ಪಿ.ಐ., ಬಾಗಲಕೋಟೆ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1434

**ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ಡಿ. ಕೃಷ್ಣಪ್ಪ, ಸಿ.ಎಚ್.ಸಿ.–133, ನರಸಾಪುರ, ಪೊಲೀಸ್ ಠಾಣೆ, ಕೋಲಾರ ಜಿಲ್ಲೆ, ಇವರು ಸರ್ಕಾರಕ್ಕೆ ಸಲ್ಲಿಸಿರುವ ಪರಿಷ್ಕರಣ ಮೇಲ್ಮನವಿ ಅರ್ಜಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:**
1) ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಕೋಲಾರ ಜಿಲ್ಲೆ ಇವರ ಆದೇಶ ಸಂಖ್ಯೆ:ಡಿಇ 08/2006–07 ಓ.ಬಿ:148/07 ದಿನಾಂಕ:27–10–2007
2) ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಕೇಂದ್ರ ವಲಯ, ಬೆಂಗಳೂರು, ಇವರ ಆದೇಶ ಸಂಖ್ಯೆ:ಅಪೀಲು 146/2008–09 ಓ.ಬಿ:38/2008–09 ದಿನಾಂಕ:06–06–08
3) ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ:31–01–09
4) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ:ಅಪೀಲು (2)106/2008–09 ದಿ:03–04–2009

**ಪ್ರಸ್ತಾವನೆ:–**

ಶ್ರೀ ಡಿ. ಕೃಷ್ಣಪ್ಪ, ಇವರು ಈ ಹಿಂದೆ ನರಸಾಪುರ ಹೊರ ಪೊಲೀಸ್ ಠಾಣೆಯಲ್ಲಿ ಸಿ.ಎಚ್.ಸಿ. ಆಗಿ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಅತೀವ ದುರ್ನಡತೆ ಹಾಗೂ ಗಂಭೀರ ಸ್ವರೂಪದ ಅಶಿಸ್ತನ್ನು ಪ್ರದರ್ಶಿಸಿದ ಕಾರಣದ ಮೇಲೆ ಇವರ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿಗಳು) ನಿಯಮಾವಳಿ 1965ರ ನಿಯಮ 6 ರಡಿ ಇಲಾಖಾ ವಿಚಾಣೆಗೆ ಆದೇಶಿಸಿ, ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷರೋಪಣೆ:–**

1. "ಶ್ರೀ.ಕೃಷ್ಣಪ್ಪ, ಸಿ.ಎಚ್.ಸಿ.–133, (ಹಾಲಿ ಅಮಾನತ್ತು) ಆದ ನೀವು ಈ ಹಿಂದೆ ನರಸಾಪುರ ಹೊರ ಪೊಲೀಸ್ ಠಾಣೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದ ಸಮಯದಲ್ಲಿ ನರಸಾಪುರ ಗ್ರಾಮದ ಶ್ರೀ.ಅಣ್ಣಿಗಿರಿಯಪ್ಪ ಬಿನ್ ಲೇಟ್ ಮುನಿಯಪ್ಪ ಎಂಬುವರ ಮನೆಯಲ್ಲಿ ಬಾಡಿಗೆಗೆ ವಾಸವಾಗಿದ್ದು, ನೀವು ವಾಸವಿದ್ದ ಎದುರು ಮನೆ ಶ್ರೀ.ಪಿಳ್ಳಪ್ಪ ಬಿನ್ ಲೇಟ್ ಮುನಿಯಪ್ಪ ಎಂಬುವರ ಮನೆಯಲ್ಲಿ ನರಸಾಪುರ ಗ್ರಾಮದ ಬಿ.ಆರ್.ಎಂ.ವಿ.ಪ್ರೌಢಶಾಲೆಯಲ್ಲಿ ವೃತ್ತಿ ಶಿಕ್ಷಕರಾಗಿ ಕರ್ತವ್ಯ ನಿರ್ವಹಿಸುತ್ತಿರುವ ಶ್ರೀ.ಪಿ.ರಾಜಣ್ಣ ಬಿನ್ ಲೇಟ್ ಪಿಳ್ಳಪ್ಪ ಎಂಬುವರು ತನ್ನ ಪತ್ನಿಯಾದ ಶ್ರೀಮತಿ.ಸುನಂದಮ್ಮ ಎಂಬಾಕೆಯೊಂದಿಗೆ ವಾಸವಾಗಿದ್ದರು. ನೀವು ವೃತ್ತಿ ಶಿಕ್ಷಕ ರಾಜಣ್ಣ ರವರ ಪತ್ನಿ ಶ್ರೀಮತಿ.ಸುನಂದಮ್ಮ, ರವರ ಜೊತೆ ಅನೈತಿಕ ಸಂಬಂಧ ಬೆಳೆಸಿಕೊಂಡು ದಿ:07–01–07 ರಂದು ರಾತ್ರಿ ಸುಮಾರು 01.30 ಗಂಟೆ ಸಮಯದಲ್ಲಿ ರಾಜಣ್ಣ ರವರು ಮನೆಯಲ್ಲಿ ಇಲ್ಲದ ವೇಳೆಯಲ್ಲಿ ಅವರ ಮನೆಗೆ ಹೋಗಿ ರಾಜಣ್ಣನ ಪತ್ನಿ ಶ್ರೀಮತಿ. ಸುನಂದಮ್ಮ ರವರ ಜೊತೆಯಲ್ಲಿ ಅನೈತಿಕ ಚಟುವಟಿಕೆಯಲ್ಲಿ ತೊಡಗಿದ್ದು, ಆ ಸಮಯದಲ್ಲಿ ರಾಜಣ್ಣ ರವರು ಕಿಟಕಿಯಲ್ಲಿ ನೋಡಿ ಮನೆ ಮುಂಬಾಗಿಲಿನ ಚಿಲಕವನ್ನು ಹಾಕಿದ್ದು, ಆಗ ಶ್ರೀಮತಿ.ಸುನಂದಮ್ಮ, ರವರು ರಾಜಣ್ಣ ರವರನ್ನು ಉದ್ದೇಶಿಸಿ ನಿಮ್ಮನ್ನು (ಕೃಷ್ಣಪ್ಪನನ್ನು) ಹೊರಗೆ ಬಿಡದಿದ್ದರೆ ತಾನು ಸೀಮೆಎಣ್ಣೆ ಹಾಕಿಕೊಂಡು ಪ್ರಾಣ ಬಿಡುತ್ತೇನೆಂದು ಬೆದರಿಕೆ ಹಾಕಿರುತ್ತಾರೆ. ನಂತರ ರಾಜಣ್ಣ, ರವರು ಊರಿನವರನ್ನು ಮತ್ತು ಪೊಲೀಸರನ್ನು ಸ್ಥಳಕ್ಕೆ ಕರೆಯಿಸಿದ್ದು, ಆಗ ನೀವು ಸ್ಥಳದಿಂದ ಹೊರಟು ಹೋಗಿ, ಅತೀವ ದುರ್ನಡತೆ ಹಾಗೂ ಗಂಭೀರ ಸ್ವರೂಪದ ಅಶಿಸ್ತನ್ನು ಪ್ರದರ್ಶಿಸಿರುವ ಬಗ್ಗೆ. "
2. "ಶ್ರೀ.ಡಿ.ಕೃಷ್ಣಪ್ಪ, ಸಿ.ಎಚ್.ಸಿ.–133, (ಹಾಲಿ ಅಮಾನತ್ತು) ಆದ ನೀವು ಈ ಹಿಂದೆ ನರಸಾಪುರ ಹೊರ ಪೊಲೀಸ್ ಠಾಣೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಮೇಲ್ಕಂಡ ಘಟನೆಗೆ ಸಂಬಂಧಪಟ್ಟಂತೆ ಶ್ರೀ.ರಾಜಣ್ಣ ಬಿನ್ ಲೇಟ್ ಪಿಳ್ಳಪ್ಪ ರವರು ನ್ಯಾಯ ದೊರಕಿಸಿಕೊಡುವಂತೆ ಕೋರಿ ದಿ:08–01–07 ರಂದು ನಿಮ್ಮ ವಿರುದ್ಧ ವೇಮಗಲ್ ಪೊಲೀಸ್ ಠಾಣೆಯಲ್ಲಿ ದೂರು ಸಲ್ಲಿಸಿದ್ದು, ಈ ಬಗ್ಗೆ ವೇಮಗಲ್ ಪೊಲೀಸ್ ಠಾಣೆಯಲ್ಲಿ ಮೊ.ಸಂ:04/2007 ಕಲಂ 497 ಐ.ಪಿ.ಸಿ. ರೀತ್ಯಾ ಪ್ರಕರಣ ದಾಖಲಾಗಿರುತ್ತದೆ. ನೀವು ಒಬ್ಬ ಜವಾಬ್ದಾರಿಯುತ ಪೊಲೀಸ್ ಅಧಿಕಾರಿಯಾಗಿದ್ದು, ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಸಾರ್ವಜನಿಕರ ಆಸ್ತಿಯ ರಕ್ಷಣೆ ಹಾಗೂ ಮಾನ ಪ್ರಾಣವನ್ನು ಕಾಪಾಡಬೇಕಾದವರೆ ತನ್ಮೂಲಕ ನೀವು ಕಾನೂನು ಬಾಹಿರ ಚಟುವಟಿಕೆ ಗಳಲ್ಲಿ ತೊಡಗಿ ಅನುಚಿತ ರೀತಿಯಲ್ಲಿ ವರ್ತಿಸಿ ಅತೀವ ದುರ್ನಡತೆ ಹಾಗೂ ಗಂಭೀರ ಸ್ವರೂಪದ ಅಶಿಸ್ತನ್ನು ಪ್ರದರ್ಶಿಸಿರುವ ಬಗ್ಗೆ. "

ಮೇಲ್ಕಂಡ ಆರೋಪದ ಮೇಲೆ ಇಲಾಖಾ ವಿಚಾರಣೆ ನಡೆಸಿ, ವಿಚಾರಣಾಧಿಕಾರಿಗಳು ಆರೋಪ ಸಾಬೀತಾಗಿದೆ ಎಂದು ಸಲ್ಲಿಸಿದ ವರದಿ ಆಧಾರದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಕೋಲಾರ ಜಿಲ್ಲೆ, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 27–10–07ರ ಆದೇಶದಲ್ಲಿ "ಅರ್ಜಿದಾರರ ಸೇವೆಯಿಂದ ವಜಾಗೊಳಿಸಲಾಗಿದೆ, ಹಾಗೂ ದಿ:09–01–07 ರಿಂದ 02–07–2007ರ ವರೆಗಿನ ಅಮಾನತ್ತಿನ ಅವಧಿಯನ್ನು ಅಮಾನತ್ತೆಂದೇ ಪರಿಗಣಿಸುವ ದಂಡನೆ ವಿಧಿಸಿರುತ್ತಾರೆ."

ಈ ಆದೇಶದ ವಿರುದ್ದ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಕೇಂದ್ರ ವಲಯ, ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ:(2)ರಲ್ಲಿ ಓದಲಾದ ದಿನಾಂಕ:06–06–08ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನೂ, ಇಲಾಖಾ ವಿಚಾರಣೆ ದಾಖಲೆಗಳನ್ನು ಪರಿಶೀಲಿಸಲಾಗಿದೆ. ಇವರ ವಿರುದ್ಧದ ಇಲಾಖಾ ವಿಚಾರಣೆಯಲ್ಲಿ ಆರೋಪ ಸಾಬೀತಾಗಿದ್ದು, ಪರಿಷ್ಕರಣ ಮೇಲ್ಮನವಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಅತೀವ ದುರ್ನಡತೆ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ, ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವೆಂದು ಪರಿಗಣಿಸುತ್ತಾ, ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಒಇ 10 ಪೊಸಿಅ 2009 ಬೆಂಗಳೂರು, ದಿನಾಂಕ: 29ನೇ ಮೇ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಡಿ. ಕೃಷ್ಣಪ್ಪ, ಮಾಜಿ ಸಿ.ಎಚ್.ಸಿ.–133, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1435

**ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ಝೇವಿಯರ್, ಎ.ಎಸ್.ಐ., ತೆಕ್ಕಲಕೋಟ ಪೊಲೀಸ್ ಠಾಣೆ, ಇವರು ಸರ್ಕಾರಕ್ಕೆ ಸಲ್ಲಿಸಿರುವ ಪರಿಷ್ಕರಣ ಮೇಲ್ಮನವಿ ಅರ್ಜಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:**
1) ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಬಳ್ಳಾರಿ, ಇವರ ಆದೇಶ ಸಂಖ್ಯೆ:17/ಇವಿ/2007 ಜಿ.ಆ. ಸಂ:872/07–08 ದಿ:31–03–2008
2) ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಪೂರ್ವ ವಲಯ, ದಾವಣಗೆರೆ ಇವರ ಆದೇಶ ಸಂಖ್ಯೆ:ಅಪೀಲು/ಸಿಬ್ಬಂದಿ–2/2008–09 ಓ.ಬಿ:85/2008–09 ದಿನಾಂಕ:29–07–08
3) ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ:24–10–08
4) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ:ಅಪೀಲು(2)100/2008–09 ದಿ:04–04–2009

**ಪ್ರಸ್ತಾವನೆ:–**

ಶ್ರೀ ಝೇವಿಯರ್, ಎ.ಎಸ್.ಐ., ಇವರು ಬಳ್ಳಾರಿ ಸಂಚಾರಿ ಪೊಲೀಸ್ ಠಾಣೆಯಲ್ಲಿ ಓ.ಓ.ಡಿ. ಆಧಾರದ ಮೇಲೆ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯದಲ್ಲಿ ಅತೀ ದುರ್ನಡತೆ ಮತ್ತು ಅಪ್ರಮಾಣಿಕತನ ಪ್ರದರ್ಶಿಸಿದ ಕಾರಣದ ಮೇಲೆ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿಗಳು) ನಿಯಮಾವಳಿ 1965ರ ನಿಯಮ 6 ರಡಿ ಇಲಾಖಾ ವಿಚಾಣೆಗೆ ಆದೇಶಿಸಿ, ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷರೋಪಣೆ:–**

1. ನೀವು ಶಿಸ್ತಿನ ಇಲಾಖೆಯಲ್ಲಿ ಕೆಲಸ ಮಾಡುತ್ತಾ, ಸಾರ್ವಜನಿಕ ಸ್ಥಳದಲ್ಲಿ ಕರ್ತವ್ಯ ನಿರ್ವಹಿಸುವಾಗ ಸಾರ್ವಜನಿಕರೊಂದಿಗೆ ಸೌಮ್ಯವಾಗಿ ವರ್ತಿಸದೇ ಶ್ರೀ.ಎಂ.ಸುದರ್ಶನಂ ಇವರೊಂದಿಗೆ ಕಟುವಾಗಿ ವರ್ತಿಸಿ ಅಂದರೆ ಅವರ ವಾಹನ ಕಳ್ಳತನದ್ದು, ಅವರು ಕಳ್ಳರು ಎನ್ನುವ ರೀತಿಯಲ್ಲಿ ಅವರಿಗೆ ಅಪಮಾನ ಮಾಡುವ ಮೂಲಕ ನಿಮ್ಮ ಕರ್ತವ್ಯದಲ್ಲಿ ಅತೀ ದುರ್ನಡತೆ ತೋರಿಸಿರುತ್ತೀರೆಂದು ಆಪಾದಿಸಲಾಗಿದೆ.

2. ನೀವು ಪೊಲೀಸ್ ಅಧಿಕಾರಿಯಾಗಿ ಪ್ರಮಾಣಿಕವಾಗಿ ಕರ್ತವ್ಯ ನಿರ್ವಹಿಸದೇ ವಾಹನ ಚಾಲಕರಾದ ಶ್ರೀ ಎಂ.ಸುದರ್ಶನಂ ಇವರಿಗೆ ಹಣ ನೀಡಿ ಸರಿ ಮಾಡಿಕೊಳ್ಳುವಂತೆ ಬೇರೊಬ್ಬರಿಂದ ಹೇಳಿಸುವ ಮೂಲಕ ಕರ್ತವ್ಯದಲ್ಲಿ ಅಪ್ರಮಾಣಿಕತನ ತೋರಿರುತ್ತೀರೆಂದು ಅಪಾದನೆ.

ಮೇಲ್ಕಂಡ ಆರೋಪದ ಮೇಲೆ ಇಲಾಖಾ ವಿಚಾರಣೆ ನಡೆಸಿ, ವಿಚಾರಣಾಧಿಕಾರಿಗಳು ಆರೋಪ (1) ಸಾಬೀತಾಗಿದೆ ಎಂದು ಸಲ್ಲಿಸಿದ ವರದಿ ಆಧಾರದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಬಳ್ಳಾರಿ, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ:31–03–08ರ ಆದೇಶದಲ್ಲಿ "ಅರ್ಜಿದಾರರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ಆರು ತಿಂಗಳ ಕಾಲ ಮುಂದಿನ ವಾರ್ಷಿಕ ವೇತನ ಬಡ್ತಿಗಳ ಮೇಲೆ ಪರಿಣಾಮ ಬೀರದಂತೆ ತಡೆಹಿಡಿದು, ದಿ:18–05–07 ರಿಂದ 27–07–2007 ರವರೆಗಿನ ಅಮಾನತ್ತಿನ ಅವಧಿಯನ್ನು ಅಮಾನತ್ತೆಂದೆ ಪರಿಗಣಿಸಿದ್ದಾರೆ."

ಈ ಆದೇಶದ ವಿರುದ್ದ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಪೂರ್ವ ವಲಯ, ದಾವಣಗೆರೆ, ಇವರು ಶಿಸ್ತುಪ್ರಾಧಿಕಾರದ ಆದೇಶವನ್ನು ಭಾಗಶ: ಪರಿಷ್ಕರಿಸಿ ಇವರ ಒಂದು ವಾರ್ಷಿಕ ವೇತನ ಬಡ್ತಿಯನ್ನು ಒಂದು ವರ್ಷಕಾಲ ಮುಂದಿನ ವೇತನ ಬಡ್ತಿಗಳಿಗೆ ದಕ್ಕೆಯಾಗದಂತೆ ಮುಂದೂಡಿ ಅಮಾನತ್ತಿನ ಅವಧಿಯನ್ನು ಅರ್ಹರಜೆಯೆಂದು ಮೇಲೆ ಕ್ರಮ ಸಂಖ್ಯೆ:(2)ರಲ್ಲಿ ಓದಲಾದ ದಿನಾಂಕ:29.07.08ರ ಆದೇಶದಲ್ಲಿ ಪರಿಗಣಿಸಿದ್ದಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನೂ, ಇಲಾಖಾ ವಿಚಾರಣೆ ದಾಖಲೆಗಳನ್ನು ಪರಿಶೀಲಿಸಲಾಗಿದೆ. ಪರಿಷ್ಕರಣ ಮೇಲ್ಮನವಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಅತೀವ ನಿರ್ಲಕ್ಷತೆ, ದುರ್ನಡತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಒಇ 382 ಪೊಸಿಅ 2008 ಬೆಂಗಳೂರು, ದಿನಾಂಕ: 3ನೇ ಜೂನ್ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಝೇವಿಯರ್, ಎ.ಎಸ್.ಐ., ತೆಕ್ಕಲಕೋಟ ಪೊಲೀಸ್ ಠಾಣೆ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1436

**ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ಎಸ್.ವೈ. ಐಹೊಳೆ, ಮಾಜಿ ಎ.ಪಿ.ಸಿ., ಡಿ.ಎ.ಆರ್., ಗದಗ, ಇವರು ಸರ್ಕಾರಕ್ಕೆ ಸಲ್ಲಿಸಿರುವ ಪರಿಷ್ಕರಣ ಮೇಲ್ಮನವಿ ಅರ್ಜಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:** 1) ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಗದಗ, ಇವರ ಆದೇಶ ಸಂಖ್ಯೆ:ಡಿಇ/ಪಿಆರ್–6/16/2004 ಅ.ಪು.ಸಂ:33/ 2005 ದಿ:31–03–2005

2) ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಉತ್ತರ ವಲಯ, ಬೆಳಗಾವಿ, ಇವರ ಆದೇಶ ಸಂಖ್ಯೆ:ಅಪೀಲು/14/ಉವ/2008–09 ದಿನಾಂಕ:17–09–08

3) ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ:26–11–08

4) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)101/08–09 ದಿ:18–04–2009

**ಪ್ರಸ್ತಾವನೆ:–**

ಶ್ರೀ ಎಸ್.ವೈ. ಐಹೊಳೆ, ಇವರು ಜಿಲ್ಲಾ ಸಶಸ್ತ್ರ ಪಡೆ, ಗದಗನಲ್ಲಿ ಸಶಸ್ತ್ರ ಪೊಲೀಸ್ ಪೇದೆ ಆಗಿ ಕರ್ತವ್ಯ ನಿರ್ವಹಿಸುತ್ತಿದ್ದಾಗ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿಗಳು) ನಿಯಮಾವಳಿ 1965ರ ನಿಯಮ 6 ರಡಿ ಇಲಾಖಾ ವಿಚಾರಣೆಗೆ ಆದೇಶಿಸಿ, ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷರೋಪಣೆ:–**

1. ನೀವು ಗದಗ ಜಿಲ್ಲಾ ಖಜಾನೆಯ ಗಾರ್ಡ್ ಕರ್ತವ್ಯ ದಲ್ಲಿದ್ದಾಗ ದಿ:06–11–2003 ರಿಂದ ಕರ್ತವ್ಯಕ್ಕೆ ಗೈರು ಹಾಜರ ಉಳಿದಿರುತ್ತೀರಿ. ನಿಮ್ಮ ಗೈರು ಹಾಜರಾತಿ ಅವಧಿಯಲ್ಲಿ ನೀವು ಮೇಲಾಧಿಕಾರಿಗಳಿಗೆ ಯಾವುದೇ ಮಾಹಿತಿ ನೀಡಿರುವುದಿಲ್ಲ ಹಾಗೂ ರಜೆ ಮಂಜೂರಾತಿಗಾಗಿ ಅರ್ಜಿಯನ್ನು

ಸಲ್ಲಿಸಿರುವುದಿಲ್ಲ ಅಲ್ಲದೇ ನೀವು ಕರ್ತವ್ಯಕ್ಕೆ ಗೈರುಹಾಜರ ಉಳಿದು 21 ದಿವಸಗಳ ಕಾಲ ಅನಧಿಕೃತ ಗೈರುಹಾಜರ ಉಳಿದಿದ್ದರಿಂದ ನಿಮಗೆ ಪೊಲೀಸ್ ಮ್ಯಾನುಯಲ್ ಆದೇಶ ಸಂಖ್ಯೆ:535ನೇದ್ದರ ಮೇರೆಗೆ ಈ ಕಛೇರಿಯಿಂದ ದಿ:03–12–2003 ರಂದು ಕರ್ತವ್ಯ ಪಲಾಯನ ಪತ್ರವನ್ನು ಜಾರಿ ಕುರಿತು ಕಳುಹಿಸಿದ್ದು, ಅದನ್ನು ಸ್ವೀಕರಿಸಿ ನೀವು ದಿ:08–12–2003ರ ವರೆಗೆ ಕರ್ತವ್ಯಕ್ಕೆ ಗೈರುಹಾಜರ ಉಳಿದು ನಿಮ್ಮ ಕರ್ತವ್ಯದಲ್ಲಿ ನಿರ್ಲಕ್ಷತನ ಹಾಗೂ ಕರ್ತವ್ಯಚ್ಯುತಿಗೈದಿದ್ದೀರಿ.

2. ನಿಮ್ಮ ಈ ಹಿಂದಿನ ಸೇವೆಯನ್ನು ಪರಿಶೀಲಿಸಿದ್ದರಲ್ಲಿ ನೀವು ದಿ:15–04–2002 ರಿಂದ 21–04–2002 ರವರೆಗೆ 7 ದಿವಸಗಳು, ದಿ:26–05–2002 ರಿಂದ 12–06–2002ರ ವರೆಗೆ 18 ದಿವಸಗಳು, ದಿ:27–08–2002 ರಿಂದ 06–10–2002ರ ವರೆಗೆ 41 ದಿವಸಗಳು, ದಿ:04–12–02 ರಿಂದ 28–01–2003 ರವರೆಗೆ 57 ದಿವಸಗಳು ದಿ: 11–06–2003 ರಿಂದ 13–06–03ರ ವರೆಗೆ 3 ದಿವಸಗಳ ಕಾಲ ಗೈರುಹಾಜರ ಉಳಿದಿದ್ದು, ಸದರಿ ಅವಧಿಗಳನ್ನು ವೇತನರಹಿತ ರಜೆ ಅಂತಾ ಪರಿಗಣಿಸಿ, ನಿಮಗೆ ಕರ್ತವ್ಯದಲ್ಲಿ ಸುಧಾರಿಸಿಕೊಳ್ಳಲು ಸಾಕಷ್ಟು ಕಾಲಾವಕಾಶ ನೀಡಿದರೂ ಸಹ ನಿಮ್ಮ ಪ್ರವೃತ್ತಿಯಲ್ಲಿ ಸುಧಾರಿಸಿಕೊಳ್ಳದೇ ಪುನ: ಅನಧಿಕೃತವಾಗಿ ಗೈರುಹಾಜರ ಉಳಿದು ನಿಮ್ಮ ಕರ್ತವ್ಯದಲ್ಲಿ ಘೋರ ಕರ್ತವ್ಯಚ್ಯುತಿ ಹಾಗೂ ನಿರ್ಲಕ್ಷತನ ತೋರಿದ್ದೀರಿ.

ಮೇಲ್ಕಂಡ ಆರೋಪದ ಮೇಲೆ ಇಲಾಖಾ ವಿಚಾರಣೆ ನಡೆಸಿ, ವಿಚಾರಣಾಧಿಕಾರಿಗಳು ಆರೋಪ ಸಾಬೀತಾಗಿದೆ ಎಂದು ಸಲ್ಲಿಸಿದ ವರದಿ ಆಧಾರದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಗದಗ, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ:31–03–05ರ ಆದೇಶದಲ್ಲಿ ಅರ್ಜಿದಾರರನ್ನು ಸೇವೆಯಿಂದ ವಜಾಗೊಳಿಸುವ ದಂಡನೆಯನ್ನು ವಿಧಿಸಿ, ದಿ:06–11–03 ರಿಂದ 08–12–02003ರ ವರೆಗೆ ಅನಧಿಕೃತವಾಗಿ ಗೈರುಹಾಜರಾದ ಅವಧಿಯನ್ನು ವೇತನರಹಿತ ರಜೆ ಎಂದು ಪರಿಗಣಿಸಿದ್ದಾರೆ.

ಈ ಆದೇಶದ ವಿರುದ್ದ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಉತ್ತರ ವಲಯ, ಬೆಳಗಾವಿ, ಇವರು ಮೇಲೆ ಕ್ರಮ ಸಂಖ್ಯೆ:(2)ರಲ್ಲಿ ಓದಲಾದ ದಿನಾಂಕ:17–09–08ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನೂ, ಇಲಾಖಾ ವಿಚಾರಣೆ ದಾಖಲೆಗಳನ್ನು ಪರಿಶೀಲಿಸಲಾಗಿದೆ. ಇವರ ವಿರುದ್ಧದ ಆರೋಪವು ಸಾಬೀತಾಗಿದ್ದು, ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪುರಸ್ಕರಿಸುವ ಸಮರ್ಥನೀಯ ಅಂಶಗಳು ಯಾವುದು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಅತೀವ ನಿರ್ಲಕ್ಷತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ, ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವೆಂದು ಪರಿಗಣಿಸುತ್ತಾ, ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಒಇ 383 ಪೊಸಿಅ 2008 ಬೆಂಗಳೂರು, ದಿನಾಂಕ: 17ನೇ ಜೂನ್ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಎಸ್.ವೈ. ಐಹೊಳೆ, ಮಾಜಿ ಎ.ಪಿ.ಸಿ., ಡಿ.ಎ.ಆರ್., ಗದಗ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1437

**ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ಗಣಪತಿರಾವ್, ಸಿ.ಎಚ್.ಸಿ.–559, ಭದ್ರಾವತಿ ಗ್ರಾಮಾಂತರ ಪೊಲೀಸ್ ಠಾಣೆ, ಶಿವಮೊಗ್ಗ, ಇವರು ಸರ್ಕಾರಕ್ಕೆ ಸಲ್ಲಿಸಿರುವ ಪರಿಷ್ಕರಣ ಮೇಲ್ಮನವಿ ಅರ್ಜಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:**
1) ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಶಿವಮೊಗ್ಗ, ಇವರ ಆದೇಶ ಸಂಖ್ಯೆ: ಸಿಬ್ಬಂದಿ(4)ಶಿಕ್ಷೆ41/08 ಓ.ಬಿ:199/08 ದಿ:27–07–2008
2) ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಪೂರ್ವ ವಲಯ, ದಾವಣಗೆರೆ, ಇವರ ಆದೇಶ ಸಂಖ್ಯೆ:21/ಅಪೀಲು/ಸಿಬ್ಬಂದಿ/2/2008–09 ಓ.ಬಿ:191/08–09 ದಿ:13–11–08
3) ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ:16–01–2009
4) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)113/2008–09 ದಿ:21–04–2009

**ಪ್ರಸ್ತಾವನೆ:–**

ಶ್ರೀ ಗಣಪತಿರಾವ್, ಸಿ.ಎಚ್.ಸಿ.–559, ಭದ್ರಾವತಿ ಗ್ರಾಮಾಂತರ ಪೊಲೀಸ್ ಠಾಣೆ, (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಇವರು ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿದ ಕಾರಣದ ಮೇಲೆ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿಗಳು) ನಿಯಮಾವಳಿ 1965ರ ನಿಯಮ 7ರಡಿ ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷರೋಪಣೆ:–**

"ಭದ್ರಾವತಿ ಗ್ರಾಮಾಂತರ ಠಾಣೆಯಲ್ಲಿ ದಾಖಲಾದ ಗು.ನಂ: 170/07 ಕಲಂ:279, 338 ಐ.ಪಿ.ಸಿ. ಪ್ರಕರಣದಲ್ಲಿ ನೊಂದವರಿಗೆ ಪರಿಹಾರ ಪಡೆಯಲು ಫಾರಂ ನಂ:110ನ್ನು ತಕ್ಷಣ ನೀಡದೆ ಅವರಿಗೆ ಸತಾಯಿಸಿ ನಿಮ್ಮ ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತೆ ಮತ್ತು ಬೇಜವಾಬ್ದಾರಿ ಪ್ರದರ್ಶಿಸಿರುತ್ತೀರಿ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಶಿವಮೊಗ್ಗ, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 27–07–08ರ ಆದೇಶದಲ್ಲಿ ಅರ್ಜಿದಾರರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ತದನಂತರದ ವೇತನ ಬಡ್ತಿಗಳಿಗೆ ಧಕ್ಕೆಯಾಗದಂತೆ ಒಂದು ವರ್ಷಕಾಲ ಮುಂದೂಡುವ ದಂಡನೆಯನ್ನು ವಿಧಿಸಿದ್ದಾರೆ.

ಈ ಆದೇಶದ ವಿರುದ್ದ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಪೂರ್ವ ವಲಯ, ದಾವಣಗೆರೆ, ಇವರು ಶಿಸ್ತು ಪ್ರಾಧಿಕಾರದ ದಂಡನಾದೇಶವನ್ನು ಭಾಗಶ: ಮಾರ್ಪಡಿಸಿ ಇವರ ಒಂದು ವಾರ್ಷಿಕ ವೇತನ ಬಡ್ತಿಯನ್ನು ಆರು ತಿಂಗಳ ಕಾಲ ಮುಂದಿನ ವೇತನ ಬಡ್ತಿಗಳಿಗೆ ದಕ್ಕೆಯಾಗದಂತೆ ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ:13–11–08ರಲ್ಲಿ ಆದೇಶಿಸಿದ್ದಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನೂ, ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಪರಿಷ್ಕರಣ ಮೇಲ್ಮನವಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಅತೀವ ನಿರ್ಲಕ್ಷತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ, ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಒಇ 23 ಪೊಸಿಅ 2009 ಬೆಂಗಳೂರು, ದಿನಾಂಕ: 17ನೇ ಜೂನ್ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಗಣಪತಿರಾವ್, ಸಿ.ಎಚ್.ಸಿ.–559, ಭದ್ರಾವತಿ ಗ್ರಾಮಾಂತರ ಪೊಲೀಸ್ ಠಾಣೆ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1438 **ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ಟಿ.ಮಂಜುನಾಥ, ಪಿ.ಐ., ಬಳ್ಳಾರಿ ಸಂಚಾರ ಪೊಲೀಸ್ ಠಾಣೆ, ಬಳ್ಳಾರಿ, ಇವರು ಸರ್ಕಾರಕ್ಕೆ ಸಲ್ಲಿಸಿರುವ ಪರಿಷ್ಕರಣ ಮೇಲ್ಮನವಿ ಅರ್ಜಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:**
1) ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಗುಲ್ಬರ್ಗಾ, ಇವರ ಆದೇಶ ಸಂಖ್ಯೆ: ಪಿಆರ್:242:2007/ಡಿಓಬಿ ಸಂ:443/08 ದಿ:28–04–08
2) ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಈಶಾನ್ಯ ವಲಯ, ಗುಲ್ಬರ್ಗಾ, ಇವರ ಆದೇಶ ಸಂಖ್ಯೆ:ಅಪೀಲು/36/ಈವ/2008 ಅ.ಪು.ಸಂ:465/ಈವ/2008 ದಿ:29–08–08
3) ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ:10–12–08
4) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಸಿಬಿ(8)109/2008–09 ದಿನಾಂಕ:20–04–2009

**ಪ್ರಸ್ತಾವನೆ:–**

ಶ್ರೀ ಟಿ.ಮಂಜುನಾಥ, ಪಿ.ಐ., ಬಳ್ಳಾರಿ ಸಂಚಾರ ಪೊಲೀಸ್ ಠಾಣೆ, (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಇವರು ಗುಲ್ಬರ್ಗಾದ ಸದರ ಬಜಾರ ಪೊಲೀಸ್ ಠಾಣೆಯಲ್ಲಿ ಪಿ.ಎಸ್.ಐ., ಆಗಿ ಕರ್ತವ್ಯ ನಿರ್ವಹಿಸುತ್ತಿದ್ದಾಗ ಕರ್ತವ್ಯದಲ್ಲಿ ವಿಮುಖತೆ ಹಾಗೂ ನಿರ್ಲಕ್ಷತನದ ಕಾರಣದ ಮೇಲೆ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿಗಳು) ನಿಯಮಾವಳಿ 1965ರ ನಿಯಮ 7ರಡಿ ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷರೋಪಣೆ:–**

"ಸದರಿ ಬಜಾರ ಪೊಲೀಸ್ ಠಾಣೆ ಗುನ್ನೆ ಸಂ:186/2006 ಕಲಂ 324, 504, 307, ಸಹಿತ 34 ಐಪಿಸಿ ನೇದ್ದರಲ್ಲಿ ಸರಿಯಾಗಿ ತನಿಖೆ ಕೈಕೊಳ್ಳದೆ ಕಾರ್ಯ ವಿಮುಖತೆ ಹಾಗೂ ನಿರ್ಲಕ್ಷತನ ತೋರಿಸಿದರ ಬಗ್ಗೆ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಗುಲ್ಬರ್ಗಾ, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 28–04–08ರ ಆದೇಶದಲ್ಲಿ ಅರ್ಜಿದಾರರ ವಾರ್ಷಿಕ ವೇತನ ಬಡ್ತಿಯನ್ನು ಮುಂದಿನ ವಾರ್ಷಿಕ ವೇತನ ಬಡ್ತಿಗಳಿಗೆ ದಕ್ಕೆಯಾಗದಂತೆ ಎರಡು ತಿಂಗಳ ಕಾಲ ಮುಂದೂಡುವ ಶಿಕ್ಷೆ ವಿಧಿಸಿರುತ್ತಾರೆ.

ಈ ಆದೇಶದ ವಿರುದ್ದ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಈಶಾನ್ಯ ವಲಯ, ಗುಲ್ಬರ್ಗಾ, ಇವರು ಮೇಲೆ ಕ್ರಮ ಸಂಖ್ಯೆ:(2)ರಲ್ಲಿ ಓದಲಾದ ದಿನಾಂಕ:29–08–08ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನೂ, ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಪರಿಷ್ಕರಣ ಮೇಲ್ಮನವಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ನಿರ್ಲಕ್ಷತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ, ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವೆಂದು ಪರಿಗಣಿಸುತ್ತಾ, ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಒಇ 09 ಪೊಸಿಅ 2009 ಬೆಂಗಳೂರು, ದಿನಾಂಕ: 19ನೇ ಜೂನ್ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಟಿ.ಮಂಜುನಾಥ, ಪಿ.ಐ., ಬಳ್ಳಾರಿ ಸಂಚಾರ ಪೊಲೀಸ್ ಠಾಣೆ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1439 **ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ಡಿ.ಬಿ. ನೀಲಯ್ಯ, ಮಾಜಿ ಹೆಚ್.ಸಿ., ಮಾಜಿ ಪ್ರಧಾನ ಮಂತ್ರಿಗಳ ಕುಟುಂಬದ ಭದ್ರತಾ ವಿಭಾಗ, ಬೆಂಗಳೂರು, ಇವರು ಸರ್ಕಾರಕ್ಕೆ ಸಲ್ಲಿಸಿರುವ ಪರಿಷ್ಕರಣ ಮೇಲ್ಮನವಿ ಅರ್ಜಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:**
1) ಶಿಸ್ತು ಪ್ರಾಧಿಕಾರಿ ಹಾಗೂ ಉಪ ಪೊಲೀಸ್ ಕಮೀಷನರ್ ಅತಿ ಗಣ್ಯ ವ್ಯಕ್ತಿಗಳ ಭದ್ರತೆ ಮತ್ತು ಮಾಜಿ ಪ್ರಧಾನ ಮಂತ್ರಿಗಳ ಭದ್ರತಾ ವಿಭಾಗ, ಬೆಂಗಳೂರು ನಗರ, ಇವರ ಆದೇಶ ಸಂಖ್ಯೆ:33/ಡಿಇ–1/ಆರ್–6/2004 ದಿ:17–12–2005
2) ಮೇಲ್ಮನವಿ ಪ್ರಾಧಿಕಾರಿ ಹಾಗೂ ಅಪರ ಪೊಲೀಸ್ ಕಮೀಷನರ್, ಸಿ.ಎ.ಆರ್., ಬೆಂಗಳೂರು, ಇವರ ಆದೇಶ ಸಂಖ್ಯೆ:01/ಅಪೀಲು/06 ದಿ:16–01–2007
3) ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ:19–04–2007
4) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ:ಅಪೀಲು (2)24/2007–08 ದಿ:08–08–2008
5) ಕರ್ನಾಟಕ ಲೋಕ ಸೇವಾ ಆಯೋಗದ ಪತ್ರ ಸಂಖ್ಯೆ:ಪಿಎಸ್‌ಸಿ 156 ಸಿಎನ್‌ಎಸ್ 08 ದಿನಾಂಕ:18.05.2009

**ಪ್ರಸ್ತಾವನೆ:–**

ಶ್ರೀ ಡಿ.ಬಿ.ನೀಲಯ್ಯ, ಎ.ಹೆಚ್.ಸಿ.–665, ಮಾಜಿ ಪ್ರಧಾನ ಮಂತ್ರಿಗಳ ಕುಟುಂಬದ ಭದ್ರತಾ ವಿಭಾಗ, ಬೆಂಗಳೂರು, ಇವರು (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯಕ್ಕೆ ಅನಧಿಕೃತವಾಗಿ ಗೈರುಹಾಜರಾದ ಕಾರಣದ ಮೇಲೆ ಇವರ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಿಯಮಗಳು) ನಿಯಮಾವಳಿ 1965ರ ನಿಯಮ 6 ರಡಿ ಇಲಾಖಾ ವಿಚಾರಣೆಗೆ ಆದೇಶಿಸಿ, ಈ ಕೆಳಕಂಡ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷರೋಪಣೆ:–**

> "ಶ್ರೀ ಡಿ.ಬಿ.ನೀಲಯ್ಯ, ಎ.ಹೆಚ್.ಸಿ.–665, ಮಾಜಿ ಪ್ರಧಾನ ಮಂತ್ರಿಗಳ ಕುಟುಂಬದ ಭದ್ರತಾ ವಿಭಾಗ, ಬೆಂಗಳೂರು ನಗರ, ಆದ ನೀವು ದಿನಾಂಕ:23.07.2004 ರಿಂದ ಇಲ್ಲಿಯವರೆಗೆ ಕರ್ತವ್ಯಕ್ಕೆ ಅನಧಿಕೃತವಾಗಿ ಗೈರುಹಾಜರಾಗಿದ್ದು, ಕರ್ತವ್ಯಕ್ಕೆ ವರಧಿ ಮಾಡಿಕೊಂಡಿರುವುದಿಲ್ಲ. ನಿಮ್ಮ ಗೈರುಹಾಜರಾತಿಯ ಅವಧಿಯು 21 ದಿನಗಳಿಗೆ ಮೀರಿದ್ದು, ಈ ಬಗ್ಗೆ ನಿಮಗೆ ಡೆಸರ್‌ಟರ್ ನೋಟಿಸನ್ನು ದಿ:05–11–2004 ರಂದು ಜಾರಿ ಮಾಡಿದ್ದರೂ ಸಹ ನೀವು ಕರ್ತವ್ಯಕ್ಕೆ ಹಾಜರಾಗದೆ ಕರ್ನಾಟಕ ರಾಜ್ಯ ಪೊಲೀಸ್ ಮ್ಯಾನುಯಲ್ ಭಾಗ–1, ಆದೇಶ ಸಂಖ್ಯೆ:525ನ್ನು ಮೀರಿರುತ್ತೀರಿ. ನಿಮ್ಮ ಗೈರು ಹಾಜರಿಯ ಬಗ್ಗೆ ನಿಮ್ಮ ಮೇಲಾಧಿಕಾರಿಗಳಿಗೆ ಯಾವುದೇ ಮಾಹಿತಿ ನೀಡಿರುವುದಿಲ್ಲ ಹಾಗೂ ಎಂ.ಹೆಚ್.ಎಸ್. ಪುಸ್ತಕವನ್ನು ಪಡೆದಿರುವುದಿಲ್ಲ. ಈ ರೀತಿ ನಿಮ್ಮ ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷ್ಯತೆ ಮತ್ತು ಕರ್ತವ್ಯ ಲೋಪವನ್ನು ಉಂಟು ಮಾಡಿರುತ್ತೀರಿ."

ಮೇಲ್ಕಂಡ ಆರೋಪದ ಮೇಲೆ ಇಲಾಖಾ ವಿಚಾರಣೆ ನಡೆಸಿ, ವಿಚಾರಣಾಧಿಕಾರಿಗಳು ಆರೋಪ ಸಾಬೀತಾಗಿದೆ ಎಂದು ಸಲ್ಲಿಸಿದ ವರದಿ ಆಧಾರದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರಿ ಹಾಗೂ ಉಪ ಪೊಲೀಸ್ ಕಮೀಷನರ್ ಅತಿ ಗಣ್ಯ ವ್ಯಕ್ತಿಗಳ ಭದ್ರತೆ ಮತ್ತು ಮಾಜಿ ಪ್ರಧಾನ ಮಂತ್ರಿಗಳ ಭದ್ರತಾ ವಿಭಾಗ, ಬೆಂಗಳೂರು ನಗರ, ಇವರು ಮೇಲೆ ಕ್ರಮ ಸಂಖ್ಯೆ: (1)ರಲ್ಲಿ ಓದಲಾದ ದಿನಾಂಕ: 17–12–2005ರ ಆದೇಶದಲ್ಲಿ ಅರ್ಜಿದಾರರನ್ನು ಸೇವೆಯಿಂದ ವಜಾಗೊಳಿಸಿ, ಗೈರುಹಾಜರಾದ ದಿನಾಂಕ:23–07–2004 ರಿಂದ 04–01–2005ರ ಅವಧಿಯನ್ನು ಸಂಬಳರಹಿತ ರಜೆ ಎಂದು ಪರಿಗಣಿಸಿದ್ದಾರೆ.

ಈ ಆದೇಶದ ವಿರುದ್ದ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಅಪರ ಪೊಲೀಸ್ ಕಮೀಷನರ್, ಸಿ.ಎ.ಆರ್., ಬೆಂಗಳೂರು ನಗರ, ಇವರು ಮೇಲೆ ಕ್ರಮ ಸಂಖ್ಯೆ:(2) ರಲ್ಲಿ ಓದಲಾದ ದಿನಾಂಕ: 16–01–2007ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನೂ, ಇಲಾಖಾ ವಿಚಾರಣೆ ದಾಖಲೆಗಳನ್ನು ಪರಿಶೀಲಿಸಲಾಗಿದೆ. ಅರ್ಜಿದಾರರ ವಿರುದ್ಧದ ಆರೋಪವು ಸಾಬೀತಾಗಿದ್ದು, ಅರ್ಜಿದಾರರು ಸರ್ಕಾರದಲ್ಲಿ ಸಲ್ಲಿಸಿದ ಸೇವೆಯನ್ನು ಗಮನದಲ್ಲಿರಿಸಿ ಮಾನವೀಯ ದೃಷ್ಟಿಯಿಂದ ಶಿಸ್ತುಪ್ರಾಧಿಕಾರದ ದಂಡನಾದೇಶವನ್ನು ಭಾಗಶ: ಮಾರ್ಪಡಿಸಲು ಸರ್ಕಾರವು ತೀರ್ಮಾನಿಸಿ ಈ ಕುರಿತು ಕರ್ನಾಟಕ ಲೋಕಸೇವಾ ಆಯೋಗದ ಸಹಮತಿಯನ್ನು ಓದಲಾದ (5)ರ ಪತ್ರದಲ್ಲಿ ಪಡೆದು, ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಒಇ 317 ಪೊಸಿಅ 2008 ಬೆಂಗಳೂರು, ದಿನಾಂಕ: 22ನೇ ಜೂನ್ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25 ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಡಿ.ಬಿ. ನೀಲಯ್ಯ, ಮಾಜಿ ಎ.ಹೆಚ್.ಸಿ. ಇವರಿಗೆ ಶಿಸ್ತುಪ್ರಾಧಿಕಾರ ವಿಧಿಸಿದ ದಂಡನಾದೇಶವನ್ನು ಭಾಗಶ: ಮಾರ್ಪಡಿಸಿ, ಸದರಿ ದಿ:17–12–05 ರಿಂದಲೇ ಜಾರಿಗೆ ಬರುವಂತೆ ಕಡ್ಡಾಯ ನಿವೃತ್ತಿಗೊಳಿಸಿ ಆದೇಶಿಸಿದೆ. ಅರ್ಜಿದಾರರು ಅನಧಿಕೃತವಾಗಿ ಗೈರುಹಾಜರಾದ ದಿನಾಂಕ: 23–07–2004 ರಿಂದ 04–01–2005ರ ವರೆಗಿನ ಅವಧಿಯನ್ನು ವೇತನ ರಹಿತ ರಜೆಯೆಂದು ಪರಿಗಣಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1440

**ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ಕೆ.ಸಿ.ರಮೇಶ್, ಅನುಯಾಯಿ–36, 3ನೇ ಪಡೆ, ಕೆ.ಎಸ್.ಆರ್.ಪಿ., ಬೆಂಗಳೂರು, ಇವರು ಸರ್ಕಾರಕ್ಕೆ ಸಲ್ಲಿಸಿರುವ ಪರಿಷ್ಕರಣ ಮೇಲ್ಮನವಿ ಅರ್ಜಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:**
1) ಶಿಸ್ತು ಪ್ರಾಧಿಕಾರಿ ಹಾಗೂ ಕಮಾಂಡೆಂಟ್, 3ನೇ ಪಡೆ, ಕೆ.ಎಸ್.ಆರ್.ಪಿ ಬೆಂಗಳೂರು, ಇವರ ಆದೇಶ ಸಂಖ್ಯೆ:ಸಿಬ್ಬಂದಿ–4/ಡಿಇ:82/2001–02 ಓ.ಬಿ:16/2001 ದಿನಾಂಕ:21–07–2001
2) ಮೇಲ್ಮನವಿ ಪ್ರಾಧಿಕಾರಿ ಹಾಗೂ ಡೆಪ್ಯೂಟಿ ಇನ್ಸ್‌ಪೆಕ್ಟರ್ ಜನರಲ್ ಆಫ್ ಪೊಲೀಸ್, ಕೆ.ಎಸ್.ಆರ್.ಪಿ., ಬೆಂಗಳೂರು, ಇವರ ಆದೇಶ ಸಂಖ್ಯೆ: 15/ಡಿಇ/2001–02 ಓ.ಬಿ:413/2001–02 ದಿ:09–10–2001
3) ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ:08–08–2007

4) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)70/2007–08 ದಿ:20–12–2007
5) ಕರ್ನಾಟಕ ಲೋಕ ಸೇವಾ ಆಯೋಗದ ಪತ್ರ ಸಂಖ್ಯೆ:ಪಿಎಸ್‌ಸಿ 107 ಸಿಎನ್‌ಎಸ್ 08 ದಿನಾಂಕ:17.03.2009

**ಪ್ರಸ್ತಾವನೆ:–**

ಶ್ರೀ ಕೆ.ಸಿ.ರಮೇಶ್, ಅನುಯಾಯಿ–36, 3ನೇ ಪಡೆ, ಕೆ.ಎಸ್.ಆರ್.ಪಿ., ಬೆಂಗಳೂರು, (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಇವರು ಅಪರಾಧ ಮೊಕದ್ದಮೆಯಲ್ಲಿ ಭಾಗಿಯಾಗಿ ಕರ್ತವ್ಯದಲ್ಲಿ ದುರ್ನಡತೆಯನ್ನು ಪ್ರದರ್ಶಿಸಿದ ಕಾರಣದ ಮೇಲೆ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಿಯಮಗಳು) ನಿಯಮಾವಳಿ 1965ರ ನಿಯಮ 6ರಡಿ ಇಲಾಖಾ ವಿಚಾರಣೆಗೆ ಆದೇಶಿಸಿ, ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷರೋಪಣೆ:–**

"ಅನುಯಾಯಿ ಸಂಖ್ಯೆ:36 ಕೆ.ಸಿ.ರಮೇಶ, ಬ–ದಳ, 3ನೇ ಪಡೆ ಕೆ.ಎಸ್.ಆರ್.ಪಿ., ಬೆಂಗಳೂರು, ಆದ ನಿಮ್ಮ ವಿರುದ್ಧ ಆಡುಗೋಡಿ ಪೊಲೀಸ್ ಠಾಣೆಯಲ್ಲಿ ಗುನ್ನೆ ಸಂಖ್ಯೆ:300:2000 ಅಂಡರ್ ಸೆಕ್ಷನ್ 498(ಎ) ಐ.ಪಿ.ಸಿ. ರನ್ವಯ ಕೇಸು ದಾಖಲಾಗಿದ್ದು, ದಿ:16–09–2000 ರಂದು ನಿಮ್ಮನ್ನು ದಸ್ತಗಿರಿ ಮಾಡಿ ನ್ಯಾಯಾಂಗ ಬಂಧನಕ್ಕೆ ಒಳಪಡಿಸಲಾಗಿರುವುದು ಶಿಸ್ತಿನ ಪೊಲೀಸ್ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿರುವ ನಿಮ್ಮ ಅತೀವ ಅಶಿಸ್ತು ಹಾಗೂ ದುರ್ನಡತೆ ಎಂಬ ಆರೋಪವಾಗಿರುತ್ತದೆ."

ಮೇಲ್ಕಂಡ ಆರೋಪದ ಮೇಲೆ ಇಲಾಖಾ ವಿಚಾರಣೆ ನಡೆಸಿ, ವಿಚಾರಣಾಧಿಕಾರಿಗಳು ಆರೋಪ ಸಾಬೀತಾಗಿಲ್ಲವೆಂದು ಸಲ್ಲಿಸಿದ ವರದಿಯನ್ನು ಶಿಸ್ತುಪ್ರಾಧಿಕಾರವು ಒಪ್ಪದೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರಿ ಹಾಗೂ ಕಮಾಂಡೆಂಟ್, 3ನೇ ಪಡೆ, ಕೆ.ಎಸ್.ಆರ್.ಪಿ ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ:(1) ರಲ್ಲಿ ಓದಲಾದ ದಿನಾಂಕ:21–07–2001ರ ಆದೇಶದಲ್ಲಿ ಅರ್ಜಿದಾರರನ್ನು "ಸೇವೆಯಿಂದ ವಜಾಗೊಳಿಸಿ, ಅಮಾನತ್ತಿನ ಅವಧಿಯನ್ನು ಅಮಾನತ್ತೆಂದೇ ಪರಿಗಣಿಸುವ ದಂಡನೆ ವಿಧಿಸಿರುತ್ತಾರೆ."

ಈ ಆದೇಶದ ವಿರುದ್ದ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಡೆಪ್ಯೂಟಿ ಇನ್ಸ್‌ಪೆಕ್ಟರ್ ಜನರಲ್ ಆಫ್ ಪೊಲೀಸ್, ಕೆ.ಎಸ್.ಆರ್.ಪಿ., ಬೆಂಗಳೂರು, ಇವರ ಮೇಲ್ಮನವಿಯನ್ನು ಮಾನವೀಯ ದೃಷ್ಟಿಯಿಂದ ಪರಿಗಣಿಸಿ, ಶಿಸ್ತುಪ್ರಾಧಿಕಾರದ ದಂಡನಾದೇಶವನ್ನು ಭಾಗಶ: ಮಾರ್ಪಡಿಸಿ, ಸೇವೆಗೆ ಪುನರ್ ನೇಮಕಮಾಡಿ, ಇವರ ನಾಲ್ಕು ವಾರ್ಷಿಕ ವೇತನ ಬಿಡ್ತಿಗಳನ್ನು ಮುಂದಿನ ವಾರ್ಷಿಕ ವೇತನ ಬಡ್ತಿಗಳಿಗೆ ದಕ್ಕೆಯಾಗುವಂತೆ ಮುಂದೂಡಿ, ನಂತರ ಹೊಸದಾಗಿ ವಾರ್ಷಿಕ ವೇತನ ಬಡ್ತಿಯನ್ನು ಪಡೆಯಲು ಮತ್ತು ಅಮಾನತ್ತಿನ ಅವಧಿಯನ್ನು ಅಮಾನತ್ತೆಂದೆ ಪರಿಗಣಿಸಿ, ಸೇವೆಯಿಂದ ವಜಗೊಂಡು ಪುನರ್‌ನೇಮಕ ಹೊಂದುವವರೆಗಿನ ಅವಧಿಯನ್ನು ವೇತನರಹಿತ ರಜೆಯೆಂದು ಮೇಲೆ ಕ್ರಮ ಸಂಖ್ಯೆ:(2) ರಲ್ಲಿ ಓದಲಾದ ದಿನಾಂಕ:09–10–2001ರಲ್ಲಿ ಆದೇಶಿಸಿದ್ದಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನೂ, ಇಲಾಖಾ ವಿಚಾರಣೆ ದಾಖಲೆಗಳನ್ನು ಪರಿಶೀಲಿಸಲಾಗಿದೆ. ದಂಡನಾ ಪ್ರಮಾಣವು ಆರೋಪಕ್ಕೆ ಅನುಗುಣವಾಗಿಲ್ಲವೆಂದು ಸರ್ಕಾರವು ಮನಗಂಡು ಈ ಕುರಿತು ಕರ್ನಾಟಕ ಲೋಕ ಸೇವಾ ಆಯೋಗದ ಸಹಮತಿಯನ್ನು ಓದಲಾದ (5)ರ ಪತ್ರದಲ್ಲಿ ಪಡೆದು ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಒಇ 11 ಪೊಸಿಅ 2008 ಬೆಂಗಳೂರು, ದಿನಾಂಕ: 20ನೇ ಮೇ 2005**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25(2)(ಬಿ) ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಕೆ.ಸಿ.ರಮೇಶ್, ಅನುಯಾಯಿ–36, 3ನೇ ಪಡೆ, ಕೆ.ಎಸ್.ಆರ್.ಪಿ., ಬೆಂಗಳೂರು, ಇವರಿಗೆ ಮೇಲ್ಮನವಿ ಪ್ರಾಧಿಕಾರವು ವಿಧಿಸಿದ ದಂಡನೆಯನ್ನು ಭಾಗಶ: ಮಾರ್ಪಡಿಸಿ, ಇವರ ಎರಡು ವಾರ್ಷಿಕ ವೇತನ ಬಡ್ತಿಗಳನ್ನು ಮುಂದಿನ ವಾರ್ಷಿಕ ವೇತನ ಬಡ್ತಿಗಳಿಗೆ ದಕ್ಕೆಯಾಗದಂತೆ ಎರಡು ವರ್ಷಗಳ ಕಾಲ ಮುಂದೂಡಿ, ಅಮಾನತ್ತಿನ ಅವಧಿಯನ್ನು ಅಮಾನತ್ತೆಂದೆ ಪರಿಗಣಿಸಿ ಸೇವೆಯಿಂದ ವಜಾಗೊಂಡು ನಂತರ ಸೇವೆಗೆ ಪುನರ್ ನೇಮಕಗೊಂಡ ಅವಧಿಯನ್ನು ಲೆಕ್ಕಕ್ಕಿಲ್ಲದ ಅವಧಿ (Dies-non) ಎಂದು ಪರಿಗಣಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1452

**ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ಸೇತುಮಾಧವನ್ ನಾಯರ್, ಪಿ.ಎಸ್.ಐ., ನಗರ ವಿಶೇಷ ಶಾಖೆ, ಬೆಂಗಳೂರು, ಇವರು ಸರ್ಕಾರಕ್ಕೆ ಸಲ್ಲಿಸಿರುವ ಪರಿಷ್ಕರಣ ಮೇಲ್ಮನವಿ ಅರ್ಜಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:** 1) ಶಿಸ್ತು ಪ್ರಾಧಿಕಾರಿ ಹಾಗೂ ಪೊಲೀಸ್ ಆಯುಕ್ತರು, ಬೆಂಗಳೂರು ನಗರ, ಇವರ ಆದೇಶ ಸಂಖ್ಯೆ: 30/ಡಿಇ1/ಆರ್6/2004 ದಿ:24–09–2007

2) ಮೇಲ್ಮನವಿ ಪ್ರಾಧಿಕಾರಿ ಹಾಗೂ ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಆದೇಶ ಸಂಖ್ಯೆ:ಅಪೀಲು(6)73/2007–08 ಓ.ಬಿ:19/2008–09 ದಿನಾಂಕ:17.05.2008

3) ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ:19–01–09

4) ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ:ಅಪೀಲು (2)111/2008–09 ದಿ:18–03–2009.

**ಪ್ರಸ್ತಾವನೆ:–**

ಶ್ರೀ ಸೇತುಮಾಧವನ್ ನಾಯರ್, ಪಿ.ಎಸ್.ಐ., ಇವರು ಸಿದ್ದಾಪುರ ಪೊಲೀಸ್ ಠಾಣೆ, ಬೆಂಗಳೂರಿನಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದ ಸಂದರ್ಭದಲ್ಲಿ ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತೆ ಮತ್ತು ಕರ್ತವ್ಯಲೋಪತೆಯ ಕಾರಣದ ಮೇಲೆ ಇವರ ವಿರುದ್ಧ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿಗಳು) ನಿಯಮಾವಳಿ 1965ರ ನಿಯಮ 6 ರಡಿ ಇಲಾಖಾ ವಿಚಾಣೆಗೆ ಆದೇಶಿಸಿ, ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷರೋಪಣೆ:–**

"ಶ್ರೀ ಸೇತುಮಾಧವನ್ ನಾಯರ್, ಪಿ.ಎಸ್.ಐ., ಸಿದ್ದಾಪುರ ಪೊಲೀಸ್ ಠಾಣೆ, (ಹಾಲಿ ನಗರ ವಿಶೇಷ ಶಾಖೆ) ಬೆಂಗಳೂರು ನಗರ, ಆದ ನೀವು ಜನವರಿ 2004ನೇ ಸಾಲಿನಲ್ಲಿ ಸಿದ್ದಾಪುರ ಪೊಲೀಸ್ ಠಾಣೆಯ ಪಿ.ಎಸ್.ಐ., ಆಗಿ ಕೆಲಸ ಮಾಡುತ್ತಿದ್ದ ಸಮಯದಲ್ಲಿ ದಿ:23–01–2004 ರಂದು 23.30 ಗಂಟೆಯಲ್ಲಿ ಸಿದ್ದಾಪುರ ಠಾಣೆಯ ಎ.ಎಸ್.ಐ. ಕೃಷ್ಣೇಗೌಡ, ರವರು ನೀಡಿದ ದೂರನ್ನು ಪಡೆದುಕೊಂಡು ಮೊ.ಸಂ.14/2004 ಕಲಂ.143–147–148–353–427 ಜೊತೆಗೆ 149 ಐ.ಪಿ.ಸಿ. ಪ್ರಕಾರ ಪ್ರಕರಣದ ದಾಖಲು ಮಾಡಿಕೊಂಡಿದ್ದು ಈ ಪ್ರಕರಣದ ತನಿಖೆಯಲ್ಲಿ ಈ ಕೆಳಕಂಡ ಲೋಪಗಳನ್ನು ಎಸಗಿರುತ್ತೀರಿ.

ಅ) ಮೊ.ಸಂ.14/2004ರ ಕಾನೂನು ತಕ್ಸೀರುಗಳು ಗಂಭೀರ ಸ್ವರೂಪದ ಪ್ರಕರಣಕ್ಕೆ ಸಂಬಂಧಪಟ್ಟಿದ್ದು ಪೊಲೀಸ್ ಮ್ಯಾನುಯಲ್ ಭಾಗ–2 ಆದೇಶ ಸಂಖ್ಯೆ:1215(1)(ಎಲ್) ಪ್ರಕಾರ ತುರ್ತು ವರಧಿಯನ್ನು (ಎಕ್ಸ್‌ಪ್ರೆಸ್ ರಿಪೋರ್ಟ್) ಮೇಲಾಧಿಕಾರಿಗಳಿಗೆ ಸಲ್ಲಿಸಬೇಕಾಗಿದ್ದು, ಆದರೆ ನೀವು ತುರ್ತು ವರಧಿಯನ್ನು ಸಲ್ಲಿಸದೆ ನಿಮ್ಮ ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತೆ ಮತ್ತು ಕರ್ತವ್ಯಲೋಪ ಎಸಗಿರುತ್ತೀರಿ.

ಆ) ನೀವು ಮೊ.ಸಂ.14/2004 ರಲ್ಲಿನ ಆರೋಪಿಗಳಾದ ಮುಜಾಯಿದ್ ಹಾಗೂ ಜಾವಿದ್ ಎಂಬುವವರನ್ನು ದಿನಾಂಕ: 17–02–2004 ರಂದು ದಸ್ತಗಿರಿ ಮಾಡಿದ್ದು, ದಸ್ತಗಿರಿ ಸಮಯದಲ್ಲಿ ನಿಮ್ಮ ವಶದಲ್ಲಿದ್ದು ನೀವು ಸದರಿಯವರನ್ನು ಕೂಲಂಕುಶವಾಗಿ ವಿಚಾರಣೆ ಮಾಡಿ ಆರೋಪಕ್ಕೆ ಸಂಬಂಧಿಸಿದ ಉಳಿದ ಆರೋಪಿಗಳನ್ನು ಪತ್ತೆ ಮಾಡಬಹುದಾಗಿದ್ದರೂ ಉದ್ದೇಶಪೂರ್ವಕವಾಗಿ ಆರೋಪಿಗಳ ವಿಚಾರಣೆ ನಡೆಸದೆ, ಮಾಹಿತಿ ಸಂಗ್ರಹಿಸದೆ ಉಳಿದ ಆರೋಪಿಗಳು ತಲೆಮರೆಸಿ ಕೊಳ್ಳಲು ಅವಕಾಶ ಮಾಡಿಕೊಟ್ಟು ನಿಮ್ಮ ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತೆ, ಕರ್ತವ್ಯಲೋಪ ಮತ್ತು ಅಸಮರ್ಪಕ ತನಿಖೆಯನ್ನು ನಡೆಸಿರುತ್ತೀರಿ.

ಇ) ಮೊ.ಸಂ.14/2004ಕ್ಕೆ ಸಂಬಂಧಿಸಿದಂತೆ ಪಿರ್ಯಾದಿಯಾದ ಶ್ರೀ.ಕೃಷ್ಣೇಗೌಡ, ಎ.ಎಸ್.ಐ., ಶ್ರೀ ಕೃಷ್ಣೇಗೌಡ, ಎಚ್.ಸಿ.–1193, ಶ್ರೀ ಸುಂದರ್‌ರಾಜ್, ಎಚ್.ಸಿ.–818, ಶ್ರೀ ಸಿದ್ದರಾಜು ಪಿ.ಸಿ.–8497 ರವರುಗಳಿಗೆ ರಕ್ತಗಾಯಗಳಾಗಿದ್ದರೂ ಸಹ ಸದರಿಯವರನ್ನು ಇಲಾಜು ಬಗ್ಗೆ ವೈದ್ಯಕೀಯ ಪರೀಕ್ಷೆಗೆ ಕಳುಹಿಸದೆ ನಿಮ್ಮ ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತೆ, ಕರ್ತವ್ಯಲೋಪ ಮತ್ತು ಅಸಮರ್ಪಕ ತನಿಖೆಯನ್ನು ನಡೆಸಿರುತ್ತೀರಿ."

ಮೇಲ್ಕಂಡ ಆರೋಪದ ಮೇಲೆ ಇಲಾಖಾ ವಿಚಾರಣೆ ನಡೆಸಿ, ವಿಚಾರಣಾಧಿಕಾರಿಗಳು ಇವರ ವಿರುದ್ಧದ ಮೂರು ಆರೋಪಗಳಲ್ಲಿ ಒಂದು ಆರೋಪ ಸಾಬೀತಾಗಿರುವುದಾಗಿ ನೀಡಿದ ವರದಿಯ ಆಧಾರದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರಿ ಹಾಗೂ ಪೊಲೀಸ್ ಆಯುಕ್ತರು, ಬೆಂಗಳೂರು ನಗರ, ಇವರು ಮೇಲೆ ಕ್ರಮ

ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ:24–09–07ರ ಆದೇಶದಲ್ಲಿ ಅರ್ಜಿದಾರರ ವೇತನವನ್ನು ಪಿ.ಎಸ್.ಐ., ಹುದ್ದೆಯ ವೇತನದ ಕನಿಷ್ಠ ಮಟ್ಟಕ್ಕೆ ಒಂದು ವರ್ಷ ಕಾಲ ಮುಂದಿನ ವಾರ್ಷಿಕ ವೇತನ ಬಡ್ತಿಗಳಿಗೆ ದಕ್ಕೆಯಾಗದಂತೆ ಇಳಿಸಿ, ದಿ:14–04–04 ರಿಂದ 27–09–2004ರ ವರೆಗಿನ ಅಮಾನತ್ತಿನ ಅವಧಿಯನ್ನು ಅಮಾನತ್ತೆಂದೆ ಪರಿಗಣಿಸಿ ಆದೇಶಿಸಿದ್ದಾರೆ.

ಈ ಆದೇಶದ ವಿರುದ್ದ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರು ಶಿಸ್ತುಪ್ರಾಧಿಕಾರದ ದಂಡನಾದೇಶವನ್ನು ಭಾಗಶ: ಮಾರ್ಪಡಿಸಿ, ಇವರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ಭವಿಷ್ಯದ ವಾರ್ಷಿಕ ವೇತನ ಬಡ್ತಿಗಳಿಗೆ ದಕ್ಕೆಯಾಗದಂತೆ ಒಂದು ವರ್ಷದ ಅವಧಿಗೆ ಮುಂದೂಡಿ, ಅಮಾನತ್ತಿನ ಅವಧಿಯನ್ನು ಅಮಾನತ್ತೆಂದೇ ಪರಿಗಣಿಸಿ ಮೇಲೆ ಕ್ರಮ ಸಂಖ್ಯೆ:(2)ರಲ್ಲಿ ಓದಲಾದ ದಿನಾಂಕ:17–05–08ರ ಆದೇಶಿಸಿದ್ದಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನೂ, ಇಲಾಖಾ ವಿಚಾರಣೆ ದಾಖಲೆಗಳನ್ನು ಪರಿಶೀಲಿಸಲಾಗಿದೆ. ಪರಿಷ್ಕರಣ ಮೇಲ್ಮನವಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಅತೀವ ನಿರ್ಲಕ್ಷತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಒಇ 25 ಪೊಸಿಅ 2009 ಬೆಂಗಳೂರು, ದಿನಾಂಕ: 20ನೇ ಮೇ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಸೇತುಮಾಧವನ್ ನಾಯರ್, ಪಿ.ಎಸ್.ಐ., ನಗರ ವಿಶೇಷ ಶಾಖೆ, ಪೊಲೀಸ್ ಆಯುಕ್ತರ ಕಛೇರಿ, ಬೆಂಗಳೂರು, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1453 **ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**ವಿಷಯ:** ಪಾವಗಡ ಪೊಲೀಸ್ ಠಾಣೆ ಪ್ರಕರಣ ಸಂಖ್ಯೆ:74/01ಕ್ಕೆ ಸಂಬಂಧಿಸಿದಂತೆ ಶ್ರೀ ಎಂ.ಕೆ.ಥಾಮಸ್, ಪಿ.ಐ ಹಾಗೂ ಇತರರ ವಿರುದ್ಧದ ಜಂಟಿ ಇಲಾಖಾ ವಿಚಾರಣೆಯಲ್ಲಿ, ಅಂತಿಮ ಆದೇಶ ಹೊರಡಿಸುವ ಬಗ್ಗೆ.

**ಓದಲಾಗಿದೆ:** 1) ಸರ್ಕಾರದ ಆದೇಶ ಸಂಖ್ಯೆ:ಒಇ 221 ಪೊಸಿಪ 2006 ದಿನಾಂಕ 29–05–2006.

2) ಪೊಲೀಸ್ ಮಹಾನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು ರವರ ಕಚೇರಿ ಪತ್ರ ಸಂಖ್ಯೆ:ಸಿಬಿ(5)32:05–06 ದಿನಾಂಕ 14–02–2008.

3) ಕಾರಣ ಕೇಳುವ ನೋಟೀಸು ಸಂಖ್ಯೆ:221 ಪೊಸಿಪ 2006 ದಿನಾಂಕ 07–07–2008.

4) ಶ್ರೀ ಕೆ.ಟಿ.ಮ್ಯಾಥ್ಯೂಸ್ ಥಾಮಸ್, ಪಿ.ಐ. ರವರ ಸಮಜಾಯಿಷಿ ದಿನಾಂಕ 29–08–2008.

**ಪ್ರಸ್ತಾವನೆ:**

ಮೇಲೆ (1)ರಲ್ಲಿ ಓದಲಾದ ಆದೇಶದಲ್ಲಿ ಶ್ರೀ ಹೆಚ್.ಎಸ್.ಆಂಜನೇಯ, ಡಿ.ಎಸ್.ಪಿ, ಚಿತ್ರದುರ್ಗ ಉಪ ವಿಭಾಗ, ಶ್ರೀ ಎಂ.ಕೆ.ಥಾಮಸ್, ಪಿ.ಐ, ನಾಗರೀಕ ಹಕ್ಕು ಜಾರಿ ನಿರ್ದೇಶನಾಲಯ, ಮಂಗಳೂರು ಶ್ರೀ ಎಸ್.ಕೇಶವರಾಜು, ಸಿ.ಪಿಸಿ–415 ಮತ್ತು ಶ್ರೀ ಯಶೋಧರ, ಸಿಪಿಸಿ–873, ಪಾವಗಡ ಪೊಲೀಸ್ ಠಾಣೆ, ಈ ನಾಲ್ಕು ಅಧಿಕಾರಿಗಳು ಪಾವಗಡ ಪೊಲೀಸ್ ಠಾಣೆ ಮೊಕದ್ದಮೆ ಸಂಖ್ಯೆ:74/01 ಕಲಂ 4.5 ರಲ್ಲಿ ಸ್ಫೋಟಕ ವಸ್ತುಗಳ ಜಪ್ತಿ ಸಮಯದಲ್ಲಿ ಬಾಂಬ್ ನಿಯಂತ್ರಣ ದಳದ ಪಿ.ಎಸ್.ಐ ರವರನ್ನು ಕೂಡಲೇ ಜಪ್ತಿ ಸ್ಥಳಕ್ಕೆ ಕರೆಸಿ ಪರಿಶೀಲನೆ ಮಾಡಿರುವುದಿಲ್ಲ ಮತ್ತು ನ್ಯಾಯಾಲಯಕ್ಕೆ ಹಾಜರಾಗಿ ಸಾಕ್ಷ್ಯ ನುಡಿಯದೇ ಕರ್ತವ್ಯದಲ್ಲಿ ಬೇಜವಾಬ್ದಾರಿತನ ಮತ್ತು ಕರ್ತವ್ಯದಲ್ಲಿ ಲೋಪವೆಸಗಿರುವ ಆರೋಪಗಳ ಹಿನ್ನೆಲೆಯಲ್ಲಿ ಇವರ ವಿರುದ್ಧ ಶಿಸ್ತು ಕ್ರಮ ಜರುಗಿಸಿ, ಜಂಟಿ ಇಲಾಖಾ ವಿಚಾರಣೆಯನ್ನು ಕೆ.ಎಸ್.ಪಿ (ಡಿಪಿ) ನಿಯಮ, 1965ರ ನಿಯಮ 6, ಉಪ ನಿಯಮ 2 ಮತ್ತು 8ರ ಅಡಿಯಲ್ಲಿ ಆದೇಶಿಸಲಾಗಿತ್ತು.

ಮೇಲೆ (2)ರಲ್ಲಿ ಓದಲಾದ ಪತ್ರದಲ್ಲಿ ವಿಚಾರಣಾಧಿಕಾರಿಗಳು, ಆರೋಪಗಳ ಬಗ್ಗೆ ಪರಿಶೀಲಿಸಿ, ಸಾಕ್ಷಿಗಳು ಹಾಗೂ ಅಧಿಕಾರಿಗಳ ಹೇಳಿಕೆಗಳನ್ನು ಪಡೆದು, ವಿಚಾರಣಾ ವರದಿಯನ್ನು ಸರ್ಕಾರಕ್ಕೆ ಸಲ್ಲಿಸಿರುತ್ತಾರೆ. ವಿಚಾರಣಾಧಿಕಾರಿಗಳು ತಮ್ಮ ವರದಿಯಲ್ಲಿ 1,3 ಮತ್ತು 4ನೇ ಆರೋಪಿತ ಅಧಿಕಾರಿಗಳ ವಿರುದ್ಧ ಮಾಡಲಾಗಿರುವ ಆರೋಪಗಳು ಸಾಬೀತಾಗಿಲ್ಲವೆಂದು ವರದಿ ಮಾಡಿರುತ್ತಾರೆ. ಮುಂದುವರೆದು, 2ನೇ ಆರೋಪಿಯಾದ ಶ್ರೀ ಎಂ.ಕೆ.ಥಾಮಸ್, ಪಿ.ಐ ಇವರನ್ನು ಸುಮಾರು 6 ಬಾರಿ ವಿಚಾರಣೆಗೆ ಸಾಕ್ಷ್ಯ ನುಡಿಯಲು ಕೋರಿದ್ದರೂ ಸಹ ನ್ಯಾಯಾಲಯಕ್ಕೆ ಹಾಜರಾಗಿ ಸಾಕ್ಷ್ಯ ನುಡಿಯುವಲ್ಲಿ ವಿಫಲರಾಗಿರುವುದು ಸಾಬೀತಾಗಿರುತ್ತದೆ ಎಂದು ವಿಚಾರಣಾಧಿಕಾರಿಗಳು ತಿಳಿಸಿರುತ್ತಾರೆ. ಮುಂದುವರಿದು, ಇವರು ತಮ್ಮ ಸಾಕ್ಷ್ಯ ನುಡಿಯಲು

ನ್ಯಾಯಾಲಯಕ್ಕೆ ಹಾಜರಾಗದೆ, ಸರ್ಕಾರಿ ಅಭಿಯೋಜಕರಿಗೆ ಸಹಕರಿಸದೇ ಇದ್ದ ಕಾರಣ ಸದರಿ ನ್ಯಾಯಾಲಯದ ಪ್ರಕರಣ ಖುಲಾಸೆಯಾಗಲು ಕಾರಣರಾಗಿರುತ್ತಾರೆಂದು ಸಹ ವಿಚಾರಣಾಧಿಕಾರಿಗಳು ತಿಳಿಸಿರುತ್ತಾರೆ.

ಮೇಲೆ (3)ರಲ್ಲಿ ಓದಲಾದ ನೋಟೀಸ್‌ನಲ್ಲಿ ಆರೋಪಿತ ಅಧಿಕಾರಿಗಳ ವಿರುದ್ಧ ವಿಚಾರಣಾಧಿಕಾರಿಗಳು ಶಿಫಾರಸ್ಸು ವರದಿಯನ್ನು ಜಾರಿ ಮಾಡಿ ಅವರಿಂದ ಸಮಜಾಯಿಷಿ ಪಡೆಯಲು ಎರಡನೇ ನೋಟೀಸ್ ಜಾರಿ ಮಾಡಲಾಗಿತ್ತು. ಮೇಲೆ (4)ರಲ್ಲಿ ಓದಲಾದ ಸಮಜಾಯಿಷಿಯಲ್ಲಿ ಆರೋಪಿತ ಅಧಿಕಾರಿಯು ತಮಗೆ ಒಂದು ಬಾರಿಯ ಸಮನ್ಸ್ ಮತ್ತು ವಾರೆಂಟ್‌ಗಳನ್ನು ನೀಡಿರುವ ಬಗ್ಗೆ ಜಾರಿ ಮಾಡಿರುವ ಬಗ್ಗೆ ವಿವರಣೆ ಪಡೆದು ವಿಚಾರಣಾಧಿಕಾರಿಗಳ ನಿರ್ಧಾರ ತೆಗೆದುಕೊಳ್ಳಬೇಕಾಗಿರುತ್ತದೆ. ಹೀಗಾಗಿ ಈ ಪ್ರಕರಣದಲ್ಲಿ ಏಕಪಕ್ಷೀಯವಾಗಿ ನಿರ್ಣಯ ತೆಗೆದುಕೊಳ್ಳಲಾಗಿದೆಯಾದ್ದರಿಂದ ತಮ್ಮ ವಿರುದ್ಧದ ದೋಷಾರೋಪಣೆಯಿಂದ ಮುಕ್ತಗೊಳಿಸಲು ಕೋರಿರುತ್ತಾರೆ.

ಪ್ರಸ್ತಾವನೆ ಪರಿಶೀಲಿಸಿದೆ. ಅಧಿಕಾರಿಗಳು ನ್ಯಾಯಾಲಯಕ್ಕೆ ಹಾಜರಾಗದೆ ಪ್ರಕರಣ ಖುಲಾಸೆಯಾಗಲು ಕಾರಣರಾಗಿರುತ್ತಾರೆಂದು ವಿಚಾರಣಾಧಿಕಾರಿಗಳ ವಿಚಾರಣಾ ವರದಿಯಿಂದ ಕಂಡು ಬಂದಿದ್ದು ಪ್ರಕರಣದಲ್ಲಿನ ಆರೋಪಿಯು ಶಿಕ್ಷೆಯಿಂದ ತಪ್ಪಿಸಿ ಕೊಂಡಿರುವುದು ಗಂಭೀರವಾಗಿರುತ್ತದೆ. ಆದ್ದರಿಂದ ಈ ಕೆಳಕಂಡಂತೆ ಆದೇಶ.

**ಸರ್ಕಾರದ ಆದೇಶ ಸಂಖ್ಯೆ:ಒಇ 221 ಪೊಸಿಪ 2006, ಬೆಂಗಳೂರು, ದಿನಾಂಕ: 29ನೇ ಮೇ 2009.**

ಪ್ರಸ್ತಾವನೆಯಲ್ಲಿ ವಿವರಿಸಿದ ಹಿನ್ನೆಲೆಯಲ್ಲಿ ಶ್ರೀ ಎಂ.ಕೆ.ಥಾಮಸ್, ಪಿ.ಐ, ನಾಗರೀಕ ಹಕ್ಕು ಜಾರಿ ನಿರ್ದೇಶನಾಲಯ, ಮಂಗಳೂರು ರವರ ಮುಂದಿನ ಎರಡು ವಾರ್ಷಿಕ ಮುಂಬಡ್ತಿ ವೇತನಗಳನ್ನು ಸಂಚಿತ ಪರಿಣಾಮ ರಹಿತವಾಗಿ (without cumulative effect) ತಡೆಹಿಡಿಯುವ ದಂಡನೆಯನ್ನು ವಿಧಿಸಿದೆ. ಪ್ರಕರಣದಲ್ಲಿನ ಇತರೆ ಆರೋಪಿಗಳಾದ ಶ್ರೀ ಹೆಚ್.ಆಂಜನೇಯ, ಡಿವೈ.ಎಸ್.ಪಿ, ಚಿತ್ರದುರ್ಗ ಉಪ ವಿಭಾಗ, ಶ್ರೀ ಎಸ್.ಕೇಶವರಾಜು, ಸಿ.ಪಿಸಿ–415 ಮತ್ತು ಶ್ರೀ ಯಶೋಧರ, ಸಿಪಿಸಿ–873, ಪಾವಗಡ ಪೊಲೀಸ್ ಠಾಣೆ, ರವರುಗಳನ್ನು ಆರೋಪಗಳಿಂದ ದೋಷಮುಕ್ತರನ್ನಾಗಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1397

**ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ಜಿ.ಎಂ. ಶಿರೂರು, ನಿವೃತ್ತ ಡಿವೈ.ಎಸ್.ಪಿ. (ಸಶಸ್ತ್ರ) ಇವರ ಅಂಅನತ್ತಿನ 6 ತಿಂಗಳ ನಂತರದ ಅವಧಿಗೆ ಜೀವನಾಂಶ ಭತ್ಯೆಯನ್ನು ಶೇಕಡ 75ಕ್ಕೆ ಏರಿಸುವ ಬಗ್ಗೆ.

**ಓದಲಾಗಿದೆ:**
1. ಸರ್ಕಾರದ ಆದೇಶ ಸಂಖ್ಯೆ ಒಇ 221 ಪೊಸಿಪ 2003 ದಿನಾಂಕ 27.08.2003.
2. ಸರ್ಕಾರದ ಆದೇಶ ಸಂಖ್ಯೆ ಒಇ 221 ಪೊಸಿಪ 2003 ದಿನಾಂಕ 30.10.2004 ಮತ್ತು 30.10.2004.
3. ಸರ್ಕಾರದ ಆದೇಶ ಸಂಖ್ಯೆ ಒಇ 221 ಪೊಸಿಪ 2003 ದಿನಾಂಕ 8.8.2007.
4. ಶ್ರೀ ಜಿ.ಎಂ. ಶಿರೂರ್, ನಿವೃತ್ತ ಡಿವೈ.ಎಸ್.ಪಿ ಇವರು ದಾಖಲಿಸಿದ ಅರ್ಜಿ ಸಂಖ್ಯೆ 3558/2008ರಲ್ಲಿ ಕೆ.ಎ.ಟಿ.ನೀಡಿದ ತೀರ್ಪು ದಿನಾಂಕ:22.09.2008.
5. ಡಿ.ಜಿ. ಮತ್ತು ಐಜಿಪಿರವರ ಸರ್ಕಾರದೊಂದಿಗೆ ವ್ಯವಹರಿಸಿದ ಕೊನೆಯ ಪತ್ರ ಸಂಖ್ಯೆ ಸಿಬಿಒ(5)/9/2003–04 ದಿನಾಂಕ 21.4.2009.

**ಪ್ರಸ್ತಾವನೆ:**

ಮೇಲೆ ಓದಲಾದ (10ರಲ್ಲಿ ಕೆಳಕಂಡ ಅಧಿಕಾರಿಗಳ ವಿರುದ್ಧ ಜಂಟಿ ಇಲಾಖಾ ವಿಚಾರಣೆಯನ್ನು ಡಿಪಿ ನಿಯಮ 6 ಮತ್ತು 8ರ ಮೇರೆಗೆ ನಡೆಸಲು ಮತ್ತು ಸೇವೆಯಿಂದ ಅಮಾನತ್ತುಗೊಳಿಸಲು ಸರ್ಕಾರ ಆದೇಶವನ್ನು ಹೊರಡಿಸಲಾಗಿರುತ್ತದೆ:–

1) ಶ್ರೀ ಬಿ.ಎನ್. ಶೆಟ್ಟಣ್ಣನವರ್, ಅಂದಿನ ಪ್ರಾಂಶುಪಾಲರು, ಪೊಲೀಸ್ ತರಬೇತಿ ಶಾಲೆ, ಖಾನಾಪುರ.
2) ಶ್ರೀ ಜಿ.ಎಂ. ಶಿರೂರ್, ಡಿವೈಎಸ್‌ಪಿ, ಅಂದಿನ ಉಪ ಪ್ರಾಂಶುಪಾಲರು
3) ಶ್ರೀ ಹುಡೇದ್‌ಗೌಡರ್, ಮೀಸಲು ಪಿ.ಐ.
4) ಶ್ರೀ ಕೆ.ಐ. ದಳವಾಯಿ, ಎ.ಆರ್.ಎಸ್.ಐ.
5) ಶ್ರೀ ಬಿ.ಎಲ್. ಹಾದಿಮನಿ, ಎಹೆಚ್‌ಸಿ
6) ಶ್ರೀ ಬಿ.ಕೆ. ಠಾಕೂರ್, ಎ.ಹೆಚ್.ಸಿ.
7) ಶ್ರೀ ಹೆಚ್.ಆರ್. ಚಿನ್ನಣ್ಣಣನವರ್, ಎ.ಹೆಚ್.ಸಿ.
8) ಶ್ರೀ ಶ್ರೀಕಾಂತ್ ವಿ. ಬಾದಿ, ಎ.ಹೆಚ್.ಸಿ.
9) ಶ್ರೀ ಆರ್.ಕೆ. ನಾವಿ, ಎ.ಹೆಚ್.ಸಿ.

ಮೇಲೆ ಓದಲಾದ (2)ರ ದಿನಾಂಕ 30.10.2004ರಲ್ಲಿ ಮೇಲಿನ ಅಧಿಕಾರಿಗಳಲ್ಲಿ ಕ್ರಮ ಸಂಖ್ಯೆ 3 ರಿಂದ 9ರವರೆಗಿನ ಒಟ್ಟು 7 ಅಧಿಕಾರಿಗಳನ್ನು ಜಂಟಿ ಇಲಾಖಾ ವಿಚಾರಣೆಯನ್ನು ಕಾಯ್ದಿರಿಸಿ, ಅಮಾನತ್ತಿನಿಂದ ಬಿಡುಗಡೆಗೊಳಿಸಿ, ಸೇವೆಗೆ

ಪುನರ್ ಸ್ಥಾಪಿಸಲಾಯಿತು ಮತ್ತು ದಿನಾಂಕ 2.3.2005ರ ಸರ್ಕಾರದ ಆದೇಶದಲ್ಲಿ ಶ್ರೀ ಜಿ.ಎಂ.ಶಿರೂರ್, ಡಿವೈಎಸ್.ಪಿ. ರವರನ್ನು ಜಂಟಿ ಇಲಾಖಾ ವಿಚಾರಣೆ ಕಾಯ್ದಿರಿಸಿ ಅಮಾನತ್ತಿನಿಂದ ತೆರವುಗೊಳಿಸಿ, ಸೇವೆಯಲ್ಲಿ ಪುನರ್ ಸ್ಥಾಪಿಸಲಾಯಿತು.

ಜಂಟಿ ಇಲಾಖಾ ವಿಚಾರಣೆಯನ್ನು ನಡೆಸಿ, ವಿಚಾರಣಾಧಿಕಾರಿಗಳು ದಿನಾಂಕ 30.6.2005ರಂದು ಅಂತಿಮ ವಿಚಾರಣಾ ವರದಿಯನ್ನು ಸಲ್ಲಿಸಿದ್ದು, ಮೇಲಿನ ಕ್ರಮ ಸಂಖ್ಯೆ 1 ರಿಂದ 5 ರವರೆಗಿನ ಅಧಿಕಾರಿಗಳ ವಿರುದ್ಧ ಆರೋಪಗಳು ಸಾಬೀತಾಗಿರುತ್ತದೆ ಎಂದೂ ಮತ್ತು ಕ್ರಮ ಸಂಖ್ಯೆ 6 ರಿಂದ 9 ರವರೆಗಿನ ಅಧಿಕಾರಿಗಳ ವಿರುದ್ಧ ಆರೋಪಗಳು ಸಾಬೀತಾಗಿರುವುದಿಲ್ಲವೆಂದು ವಿಚಾರಣಾಧಿಕಾರಿಗಳು ತಮ್ಮ ವಿಚಾರಣಾ ವರದಿಯಲ್ಲಿ ತಿಳಿಸಿರುತ್ತಾರೆ. ಆದುದರಿಂದ, ಮೇಲೆ ಓದಲಾದ (3)ರ ಸರ್ಕಾರದ ಆದೇಶ ದಿನಾಂಕ 8.8.2007ರಲ್ಲಿ ಕೆಳಕಂಡ ಅಧಿಕಾರಿಗಳ ವಿರುದ್ಧದ ಆರೋಪಗಳು ಸಾಬೀತಾದ ಹಿನ್ನೆಲೆಯಲ್ಲಿ ವಿಚಾರಣಾ ವರದಿಯನ್ನು ಒಪ್ಪಿ, ಸೇವೆಯಿಂದ ಕಡ್ಡಾಯ ನಿವೃತ್ತಿಗೊಳಿಸುವ ದಂಡನೆಯನ್ನು ವಿಧಿಸಲಾಯಿತು:–

(1) ಶ್ರೀ ಹುಡೇದ್‌ಗೌಡರ್, ಆರ್.ಪಿ.ಐ.

(2) ಶ್ರೀ ಕೆ.ವಿ. ದಳವಾಯಿ, ಎ.ಆರ್.ಎಸ್.ಐ.

(3) ಶ್ರೀ ಜಿ.ಎಲ್. ಹಾದಿಮನಿ

ಶ್ರೀ ಬಿ.ಎನ್. ಶೆಟ್ಟಣ್ಣನವರ್ ಮತ್ತು ಶ್ರೀ ಜಿ.ಎನ್. ಶಿರೂರ್, ಇವರುಗಳು ಸೇವೆಯಿಂದ ನಿವೃತ್ತರಾದುದರಿಂದ, ಇವರಿಗೆ ಶೇಕಡ 50ರಷ್ಟನ್ನು ಇವರ ಪಿಂಚಣಿಯಿಂದ ಐದು ವರ್ಷಗಳ ಅವಧಿಯವರೆಗೆ ಕಡಿತಗೊಳಿಸುವ ದಂಡನೆಯನ್ನು ವಿಧಿಸಲಾಗಿದೆ.

ಮೇಲೆ ಓದಲಾದ (4)ರ ದಿನಾಂಕ 22.9.2008ರ ತೀರ್ಪಿನಲ್ಲಿ ಮಾನ್ಯ ಕೆ.ಎ.ಟಿಯು ಶ್ರೀ ಶಿರೂರ್‌ರವರನ್ನು ದಿನಾಂಕ 27.8.2003ರಂದು ಅಮಾನತ್ತಿನಲ್ಲಿರಿಸಿ, ದಿನಾಂಕ 2.3.2005ರಂದು ಇವರ ಅಮಾನತ್ತನ್ನು ತೆರವುಗೊಳಿಸಿದ್ದು, ಸದರಿ ಅಮಾನತ್ತಿನ ಆರು ತಿಂಗಳ ಅವಧಿಯ ನಂತರ ಜೀವನಾಂಶ ಭತ್ಯವನ್ನು 75ಕ್ಕೆ ಏರಿಸಬೇಕೆಂಬ ಶ್ರೀಯುತರ ಕೋರಿಕೆಯನ್ನು ಪರಿಗಣಿಸಿ, ಸೂಕ್ತ ಆದೇಶಗಳನ್ನು ಹೊರಡಿಸುವಂತೆ ತಿಳಿಸಿದೆ.

ಮಾನ್ಯ ಕೆ.ಎ.ಟಿ.ಯು ತನ್ನ ಆದೇಶ ದಿನಾಂಕ 22.9.2008ರಲ್ಲಿ ಸೂಚಿಸಿದಂತೆ, ಇವರ ಜೀವನಾಂಶ ಭತ್ಯೆಯನ್ನು ಹೆಚ್ಚಿಸುವ ಬಗ್ಗೆ ಸರ್ಕಾರ ಪರಿಶೀಲಿಸಿ, ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ ಒಇ 142 ಪೊಸಿಪ 2009, ಬೆಂಗಳೂರು, ದಿನಾಂಕ: 19ನೇ ಜೂನ್ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಶ್ರೀ ಜಿ.ಎಂ.ಶಿರೂರ್, ನಿವೃತ್ತ ಡಿವೈ.ಎಸ್.ಪಿ. (ಸಶಸ್ತ್ರ), ಇವರು ಮಾನ್ಯ ಕೆ.ಎ.ಟಿ.ಯಲ್ಲಿ ಅರ್ಜಿ ಸಂಖ್ಯೆ 3558/2008ರಲ್ಲಿ ದಿನಾಂಕ 22.9.2008ರ ತೀರ್ಪಿನಲ್ಲಿ ಸೂಚಿಸಿರುವಂತೆ, ಶ್ರೀ ಶಿರೂರ್‌ರವರನ್ನು ಅಮಾನತ್ತುಗೊಳಿಸಿದ ದಿನಾಂಕ 27.8.2003 ರಿಂದ ಆರು ತಿಂಗಳುಗಳ ಅವಧಿಯ ನಂತರದ ಅವಧಿಗೆ ಜೀವನಾಂಶ ಭತ್ಯೆಯನ್ನು ಇವರ ಅಮಾನತ್ತನ್ನು ತೆರವುಗೊಳಿಸಿದ ದಿನಾಂಕ 2.3.2005ರವರೆಗೆ ಶೇಕಡ 50 ರಿಂದ ಕೆ.ಸಿ.ಎಸ್.ಆರ್. ನಿಯಮ–98ರನ್ವಯ ಶೇಕಡ 75ಕ್ಕೆ ಏರಿಸಿ, ಆದೇಶಿಸಿದೆ. ಮುಂದುವರೆದು, ಇವರ ಅಮಾನತ್ತಿನ ಅವಧಿಯನ್ನು ಅಮಾನತ್ತೆಂದೆ ಪರಿಗಣಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1441

**ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ಸಿ.ಡಿ.ನಾಗರಾಜ್, ಪ್ರೊ.ಪಿಎಸ್ಐ, ರವರ ಖಾಯಂಪೂರ್ವ ಅವಧಿ ವಿಸ್ತರಿಸುವ ಕುರಿತು.

**ಓದಲಾಗಿದೆ:** ಡಿಜಿ ಮತ್ತು ಐಜಿಪಿ ರವರ ಪತ್ರ ಸಂಖ್ಯೆ:117/ಸಿಬ್ಬಂದಿ–1/2008–09 ದಿನಾಂಕ 28–04–2009.

**ಪ್ರಸ್ತಾವನೆ:**

ಶ್ರೀ ಸಿ.ಡಿ.ನಾಗರಾಜ್, ಪಿ.ಎಸ್.ಐ. ರವರು ದಿನಾಂಕ 30–12–2001 ರಂದು ಪಿ.ಎಸ್.ಐ. ಆಗಿ ನೇಮಕಗೊಂಡಿರುತ್ತಾರೆ. ಸದರಿಯವರು ಹುದ್ದೆಗೆ ನಿಗಧಿಪಡಿಸಿದ ಅಕೌಂಟ್ಸ್ ಹೈಯರ್ ಇಲಾಖಾ ಪರೀಕ್ಷೆಯಲ್ಲಿ ಉತ್ತೀರ್ಣರಾಗಿಲ್ಲವಾದ್ದರಿಂದ ಇವರ ಖಾಯಂ ಪೂರ್ವ ಅವಧಿಯನ್ನು ಕೆ.ಸಿ.ಎಸ್. (ಪ್ರೊಬೇಷನರಿ) ನಿಯಮಗಳು, 1977ರ ನಿಯಮ 4(1)(ii) ರನ್ವಯ 30–06–2004 ರಿಂದ 29–09–2005 ರವರೆಗೆ ಐಜಿಪಿ, ಪಶ್ಚಿಮ ವಲಯ ರವರು ವಿಸ್ತರಿಸಿರುತ್ತಾರೆ.

ಸದರಿ ಪಿ.ಎಸ್.ಐ. ರವರು ದಿನಾಂಕ 09–06–2007 ರಂದು ಅಕೌಂಟ್ಸ್ ಹೈಯರ್ ಪರೀಕ್ಷೆಯಲ್ಲಿ ಉತ್ತೀರ್ಣರಾಗಿರುವುದರಿಂದ ಹಾಗೂ ಇವರ ವಿರುದ್ಧ ಚಾಲ್ತಿ ಶಿಕ್ಷೆ / ಇಲಾಖಾ ವಿಚಾರಣೆ ಹಾಗೂ ಕ್ರಿಮಿನಲ್ ಮೊಕದ್ದಮೆಗಳು ಬಾಕಿ ಇರುವುದಿಲ್ಲವಾದ್ದರಿಂದ ಖಾಯಂ ಪೂರ್ವ ಅವಧಿಯನ್ನು ದಿನಾಂಕ 30–09–2005 ರಿಂದ 08–06–2007 ರವರೆಗೆ ವಿಸ್ತರಿಸುವಂತೆ ಡಿಜಿ ಮತ್ತು ಐಜಿಪಿ ರವರು ಮೇಲೆ ಓದಲಾದ ಪತ್ರದಲ್ಲಿ ಕೋರಲಾಗಿರುತ್ತದೆ.

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿದ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಒಇ 147 ಪೊಸಇ 2009, ಬೆಂಗಳೂರು, ದಿನಾಂಕ: 19ನೇ ಜೂನ್ 2009.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳನ್ನು ಪರಿಶೀಲಿಸಿ ಸರ್ಕಾರವು ಕರ್ನಾಟಕ ನಾಗರೀಕ ಸೇವಾ (ಪ್ರೊಬೇಷನ್) ನಿಯಮಾವಳಿಗಳು, 1977ರ ನಿಯಮ 4(1)(i) ರನ್ವಯ ಶ್ರೀ ಸಿ.ಡಿ.ನಾಗರಾಜ್, ಪಿ.ಎಸ್.ಐ. ಇವರ ಖಾಯಂ ಪೂರ್ವ ಅವಧಿಯನ್ನು ದಿನಾಂಕ 30–09–2005 ರಿಂದ 08–06–2007 ರವರೆಗೆ ವಿಸ್ತರಿಸಿ ಆದೇಶಿಸಿದೆ.

ವಿಸ್ತರಿಸಿದ ಪರಿವೀಕ್ಷಣಾ ಅವಧಿಗೆ ಕ.ನಾ.ಸೇ (ಪರಿವೀಕ್ಷಣೆ) ನಿಯಮಗಳು 1977ರ ನಿಯಮ 10ರ ಪ್ರಕಾರ ವಾರ್ಷಿಕ ವೇತನ ಬಡ್ತಿಗಳನ್ನು ನೀಡುವಂತಿಲ್ಲ. ಕಾಲ್ಪನಿಕವಾಗಿ ವಾರ್ಷಿಕ ವೇತನ ಬಡ್ತಿಗಳನ್ನು ಬಿಡುಗಡೆ ಮಾಡಿ ವೇತನವನ್ನು ನಿಗಧಿಪಡಿಸುವುದು. ಹೀಗೆ ನಿಗಧಿಪಡಿಸಿದ ವೇತನದ ಬಾಕಿಯನ್ನು ನೀಡಲು ಅವಕಾಶವಿರುವುದಿಲ್ಲ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1442

**ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**ವಿಷಯ:** ಶ್ರೀ ಬಿ.ಎನ್.ಶೆಟ್ಟಣ್ಣನವರ್, ಹಿಂದಿನ ಪ್ರಾಂಶುಪಾಲರು ಹಾಗೂ ಅಡಿಷನಲ್ ಎಸ್.ಪಿ., ಪೊಲೀಸ್ ತರಬೇತಿ ಶಾಲೆ, ಖಾನಾಪುರ ಮತ್ತಿತರರ ವಿರುದ್ಧ ಶಿಸ್ತು ಕ್ರಮ ಜರುಗಿಸುವ ಬಗ್ಗೆ.

**ಓದಲಾಗಿದೆ:** 1) ಸರ್ಕಾರದ ಆದೇಶ ಸಂಖ್ಯೆ:ಒಇ 221 ಪೊಸಿಪ 2003 ದಿನಾಂಕ 27–08–2003,
2) ಸರ್ಕಾರದ ಆದೇಶ ಸಂಖ್ಯೆ:ಒಇ 221 ಪೊಸಿಪ 2003 ದಿನಾಂಕ 30–10–2004 & 30–10–2004.
3) ಸರ್ಕಾರದ ಆದೇಶ ಸಂಖ್ಯೆ:ಒಇ 221 ಪೊಸಿಪ 2003 ದಿನಾಂಕ 08–08–2007.
4) ಡಿಜಿ ಮತ್ತು ಐಜಿಪಿ ರವರು ಸರ್ಕಾರದೊಂದಿಗೆ ವ್ಯವಹರಿಸಿದ ಕೊನೆಯ ಪತ್ರ ಸಂಖ್ಯೆ:ಸಿಬಿ(5)/9/2003–04 ದಿನಾಂಕ 21–04–2009.

**ಪ್ರಸ್ತಾವನೆ:**

ಮೇಲೆ (1) ರಲ್ಲಿ ಕೆಳಕಂಡ ಅಧಿಕಾರಿಗಳ ವಿರುದ್ಧ ಜಂಟಿ ಇಲಾಖಾ ವಿಚಾರಣೆಯನ್ನು ಕೆ.ಎಸ್.ಪಿ ಡಿಪಿ ನಿಯಮ 6 ಮತ್ತು 8ರ ಮೇರೆಗೆ ನಡೆಸಲು ಮತ್ತು ಸೇವೆಯಿಂದ ಅಮಾನತ್ತುಗೊಳಿಸಲು ಸರ್ಕಾರ ಆದೇಶವನ್ನು ಹೊರಡಿಸಲಾಗಿರುತ್ತದೆ:–

1) ಶ್ರೀ.ಜಿ.ಎನ್.ಶೆಟ್ಟಣ್ಣನವರ್, ಅಂದಿನ ಪ್ರಾಂಶುಪಾಲರು, ಪೊಲೀಸ್ ತರಬೇತಿ ಶಾಲೆ, ಖಾನಾಪುರ.
2) ಶ್ರೀ.ಜಿ.ಎನ್.ಶಿರೂರ್, ಡಿವೈ.ಎಸ್.ಪಿ. ಅಂದಿನ ಉಪ ಪ್ರಾಂಶುಪಾಲರು.
3) ಶ್ರೀ.ಹುಡೇದ್ ಗೌಡರ್, ಮೀಸಲು ಪಿ.ಐ.
4) ಶ್ರೀ.ಕೆ.ವಿ.ದಳವಾಯಿ, ಎ.ಆರ್.ಎಸ್.ಐ.
5) ಶ್ರೀ.ಜಿ.ಎಲ್.ಹಾದಿಮನಿ, ಎ.ಹೆಚ್.ಸಿ.
6) ಶ್ರೀ.ಬಿ.ಕೆ.ಠಾಕೂರ್, ಎ.ಹೆಚ್.ಸಿ.
7) ಶ್ರೀ.ಹೆಚ್.ಆರ್.ಚಿನ್ನಣ್ಣನವರ್, ಎ.ಹೆಚ್.ಸಿ.
8) ಶ್ರೀ.ಶ್ರೀಕಾಂತ ವಿ.ಬಾಧಿ, ಎ.ಹೆಚ್.ಸಿ.
9) ಶ್ರೀ.ಆರ್.ಕೆ.ನಾವಿ, ಎ.ಹೆಚ್.ಸಿ.

2) ಮೇಲೆ ಓದಲಾದ (2)ರ ಆದೇಶ ದಿನಾಂಕ 30–10–2004ರಲ್ಲಿ ಮೇಲಿನ ಅಧಿಕಾರಿಗಳಲ್ಲಿ ಕ್ರಮ ಸಂಖ್ಯೆ:3 ರಿಂದ 9ರ ವರೆಗಿನ ಒಟ್ಟು 7 ಅಧಿಕಾರಿಗಳನ್ನು ಜಂಟಿ ಇಲಾಖಾ ವಿಚಾರಣೆಯನ್ನು ಕಾಯ್ದಿರಿಸಿ, ಅಮಾನತ್ತಿನಿಂದ ಬಿಡುಗಡೆಗೊಳಿಸಿ, ಸೇವೆಗೆ ಪುನರ್ ಸ್ಥಾಪಿಸಲಾಯಿತು ಮತ್ತು ದಿನಾಂಕ 02–03–2005ರ ಸರ್ಕಾರದ ಆದೇಶದಲ್ಲಿ ಶ್ರೀ ಜಿ.ಎಂ.ಶಿರೂರ್, ಡಿವೈ.ಎಸ್.ಪಿ ರವರನ್ನು ಜಂಟಿ ಇಲಾಖಾ ವಿಚಾರಣೆ ಕಾಯ್ದಿರಿಸಿ ಅಮಾನತ್ತಿನಿಂದ ತೆರವುಗೊಳಿಸಿ, ಸೇವೆಯಲ್ಲಿ ಪುನರ್ ಸ್ಥಾಪಿಸಲಾಯಿತು.

3) ಜಂಟಿ ಇಲಾಖಾ ವಿಚಾರಣೆಯನ್ನು ನಡೆಸಿ, ವಿಚಾರಣಾಧಿಕಾರಿಗಳು ದಿನಾಂಕ 30–06–2005ರಂದು ಅಂತಿಮ ವಿಚಾರಣಾ ವರದಿಯನ್ನು ಸಲ್ಲಿಸಿದ್ದು, ಮೇಲಿನ ಕ್ರಮ ಸಂಖ್ಯೆ:1 ರಿಂದ 5 ರ ವರೆಗಿನ ಅಧಿಕಾರಿಗಳ ವಿರುದ್ಧ ಆರೋಪಗಳು ಸಾಬೀತಾಗಿರುತ್ತದೆ ಎಂದೂ ಮತ್ತು ಕ್ರಮ ಸಂಖ್ಯೆ:6 ರಿಂದ 9ರ ವರೆಗಿನ ಅಧಿಕಾರಿಗಳ ವಿರುದ್ಧ ಆರೋಪಗಳು ಸಾಬೀತಾಗಿರುವುದಿಲ್ಲವೆಂದು ವಿಚಾರಣಾಧಿಕಾರಿಗಳು ತಮ್ಮ ವಿಚಾರಣಾ ವರದಿಯಲ್ಲಿ ತಿಳಿಸಿರುತ್ತಾರೆ. ಆದುದರಿಂದ, ಮೇಲೆ ಓದಲಾದ (3)ರ ಸರ್ಕಾರದ ಆದೇಶ ದಿನಾಂಕ 08–08–2007ರಲ್ಲಿ ಕೆಳಕಂಡ ಅಧಿಕಾರಿಗಳ ವಿರುದ್ಧದ ಆರೋಪಗಳು ಸಾಬೀತಾದ ಹಿನ್ನೆಲೆಯಲ್ಲಿ ವಿಚಾರಣಾ ವರದಿಯನ್ನು ಒಪ್ಪಿ, ಸೇವೆಯಿಂದ ಕಡ್ಡಾಯ ನಿವೃತ್ತಿಗಳಿಸುವ ದಂಡನೆಯನ್ನು ವಿಧಿಸಲಾಯಿತು:–

(1) ಶ್ರೀ ಹುಡೇದ್ ಗೌಡರ್, ಆರ್.ಪಿ.ಐ.
(2) ಶ್ರೀ ಕೆ.ವಿ.ದಳವಾಯಿ, ಎ.ಆರ್.ಎಸ್.ಐ.
(3) ಶ್ರೀ ಜಿ.ಎಲ್.ಹಾದಿಮನಿ.

4) ಶ್ರೀ ಬಿ.ಎನ್.ಶೆಟ್ಟಣ್ಣನವರ್ ಮತ್ತು ಶ್ರೀ ಜಿ.ಎನ್.ಶಿರೂರ್, ಇವರುಗಳು ಸೇವೆಯಿಂದ ನಿವೃತ್ತರಾದುದರಿಂದ ಇವರಿಗೆ ಶೇಕಡ 50ರಷ್ಟನ್ನು ಇವರ ಪಿಂಚಣಿಯಿಂದ ಐದು ವರ್ಷಗಳ ಅವಧಿಯವರೆಗೆ ಕಡಿತಗೊಳಿಸುವ ದಂಡನೆಯನ್ನು ವಿಧಿಸಲಾಗಿದೆ.

5) ಮುಂದುವರಿದು, ಈ ಕೆಳಕಂಡ ಸಿಬ್ಬಂದಿಗಳ ವಿರುದ್ಧ ಇಲಾಖಾ ವಿಚಾರಣೆಯಲ್ಲಿ ಆರೋಪವು ಸಾಬೀತಾಗಿರುವುದಿಲ್ಲವೆಂದು ವರದಿ ಮಾಡಿದ ಹಿನ್ನೆಲೆಯಲ್ಲಿ ಇವರುಗಳನ್ನು ದೋಷಮುಕ್ತಗೊಳಿಸಲಾಗಿರುತ್ತದೆ:–

(1) ಶ್ರೀ ಹೆಚ್.ಆರ್.ಚಿನ್ನಣ್ಣನವರ್, ಎ.ಹೆಚ್.ಸಿ.
(2) ಶ್ರೀ ಶ್ರೀಕಾಂತ ವಿ.ಬಾಧಿ, ಎ.ಹೆಚ್.ಸಿ.
(3) ಶ್ರಿ ಆರ್.ಕೆ.ನಾವಿ, ಎ.ಹೆಚ್.ಸಿ.
(4) ಶ್ರೀ ಜಿ.ಕೆ.ಠಾಕೂರ್, ಎ.ಹೆಚ್.ಸಿ.

6) ಮೇಲೆ ಓದಲಾದ(4)ರ ತಮ್ಮ ಪತ್ರದಲ್ಲಿ ಡಿಜಿ ಮತ್ತು ಐಜಿಪಿ ರವರು ಹಿಂದಿನ ಖಂಡಿಕೆಯಲ್ಲಿ ನಮೂದಿಸಿರುವ ಅಧಿಕಾರಿಗಳ ವಿರುದ್ಧದ ಆರೋಪಗಳು ಸಾಬೀತಾಗಿಲ್ಲದೆ ಇರುವುದರಿಂದ, ಇವರುಗಳನ್ನು ಅಮಾನತ್ತುಗೊಳಿಸಿದ ದಿನಾಂಕ:27.08.2003 ರಿಂದ ಇವರುಗಳನ್ನು ಸೇವೆಗೆ ಪುನರ್ ನೇಮಿಸಿದ ದಿನಾಂಕ 30–10–2004ರ ವರೆಗಿನ ಅವಧಿಯನ್ನು ಕರ್ತವ್ಯದ ಮೇಲಿದ್ದಂತೆ ಎಂದು ಪರಿಗಣಿಸಿ ಆದೇಶ ಹೊರಡಿಸಬೇಕೆಂದು ಕೋರಿರುತ್ತಾರೆ.

7) ಡಿಜಿ ಮತ್ತು ಐಜಿಪಿ ರವರ ಪ್ರಸ್ತಾವನೆಯನ್ನು ಸರ್ಕಾರ ಪರಿಶೀಲಿಸಿ ಈ ಕೆಳಗಿನಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಒಇ 142 ಪೊಸಿಪ 2009, ಬೆಂಗಳೂರು, ದಿನಾಂಕ: 19ನೇ ಜೂನ್ 2009.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಈ ಕೆಳಕಂಡ ಪೊಲೀಸ್ ಸಿಬ್ಬಂದಿಗಳ ವಿರುದ್ಧದ ಆರೋಪಗಳು ಜಂಟಿ ಇಲಾಖಾ ವಿಚಾರಣೆಯಲ್ಲಿ ಸಾಭೀತಾಗಿರುವುದಿಲ್ಲವಾದುದರಿಂದ, ಇವರುಗಳನ್ನು ದೋಷಮುಕ್ತಗೊಳಿಸಿ ಆದೇಶಿಸಲಾಗಿದೆ ಮತ್ತು ಇವರುಗಳ ಅಮಾನತ್ತಿನ ಅವಧಿ ದಿನಾಂಕ 27–08–2003 ರಿಂದ 30–10–2004 ರ ವರೆಗಿನ ಅವಧಿಯನ್ನು **"ಕರ್ತವ್ಯದ ಅವಧಿ"** ಎಂದು ಸಹ ಪರಿಗಣಿಸಿ ಆದೇಶಿಸಲಾಗಿದೆ.

1. ಶ್ರೀ.ಹೆಚ್.ಆರ್.ಚಿನ್ನಣ್ಣನವರ್, ಎ.ಹೆಚ್.ಸಿ.
2. ಶ್ರೀ.ಶ್ರೀಕಾಂತ ವಿ.ಬಾಧಿ, ಎ.ಹೆಚ್.ಸಿ.
3. ಶ್ರೀ.ಆರ್.ಕೆ.ನಾವಿ, ಎ.ಹೆಚ್.ಸಿ.
4. ಶ್ರೀ.ಜಿ.ಕೆ.ಠಾಕೂರ್, ಎ.ಹೆಚ್.ಸಿ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1444 **ಟಿ.ಎನ್. ರವಿಪ್ರಕಾಶ್**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

## ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಸಚಿವಾಲಯ

**ವಿಷಯ:** ಕರ್ನಾಟಕ ಸರ್ಕಾರ ಸಚಿವಾಲಯದ ಜಲಸಂಪನ್ಮೂಲ ಇಲಾಖೆಯಲ್ಲಿನ ಕೃಷ್ಣಾ ಭಾಗ್ಯ ಜಲ ನಿಗಮ ವಿಶೇಷ ಕೋಶವನ್ನು ಅದರ ಹುದ್ದೆಗಳೊಂದಿಗೆ ಮುಂದುವರಿಸುವ ಬಗ್ಗೆ.

**ಓದಲಾಗಿದೆ:**
1. ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 14 ಸಸಿವಿ 1994, ದಿನಾಂಕ: 07–07–1994.
2. ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 34 ಸಸಿವಿ 1999, ದಿನಾಂಕ: 22–10–1999.
3. ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 09 ಸಸಿವಿ 2007, ದಿನಾಂಕ: 02–03–2007.
4. ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 377 ಸಅಸೇ 2008, ದಿನಾಂಕ: 15–05–2008 ಮತ್ತು ತಿದ್ದೋಲೆ ದಿನಾಂಕ: 04–06–2008.
5. ಜಲಸಂಪನ್ಮೂಲ ಇಲಾಖೆಯ ಕಡತ ಸಂಖ್ಯೆ: ಜಸಂಇ 41 ಕೆಬಿಎನ್ 08.

**ಪ್ರಸ್ತಾವನೆ:–**

ಮೇಲೆ ಓದಲಾದ (1) ಮತ್ತು (2) ರ ಸರ್ಕಾರದ ಆದೇಶಗಳಲ್ಲಿ ಕೃಷ್ಣಾ ಭಾಗ್ಯ ಜಲ ನಿಗಮದ ಪ್ರಾರಂಭಿಕ ಕಾರ್ಯಗಳನ್ನು ನಿರ್ವಹಿಸಲು ಕರ್ನಾಟಕ ಸರ್ಕಾರ ಸಚಿವಾಲಯದ ನೀರಾವರಿ ಇಲಾಖೆಯಲ್ಲಿ ಈ ಕೆಳಕಂಡ ಹುದ್ದೆಗಳನ್ನು ಒಳಗೊಂಡಂತೆ ಕೃಷ್ಣಾ ಭಾಗ್ಯ ಜಲ ನಿಗಮದ ವಿಶೇಷ ಕೋಶವನ್ನು ಒಂದು ವರ್ಷದ ಅವಧಿಗೆ ಸೃಜಿಸಲಾಗಿತ್ತು ಹಾಗೂ ವಿಶೇಷಾಧಿಕಾರಿ ಮತ್ತು ಪದನಿಮಿತ್ತ ಉಪ ಕಾರ್ಯದರ್ಶಿ, ನೀರಾವರಿ ಇಲಾಖೆ (ಕೃಷ್ಣಾ ಭಾಗ್ಯ ಜಲ ನಿಗಮ ವಿಶೇಷ ಕೋಶ) ಇವರ ಆಪ್ತ ಶಾಖೆಗೆ ಪೂರಕ ಸಿಬ್ಬಂದಿ ಹುದ್ದೆಗಳನ್ನು ಸೃಜಿಸಲಾಗಿದೆ. ಈ ತಾತ್ಕಾಲಿಕ ಹುದ್ದೆಗಳನ್ನು ಕಾಲಕಾಲಕ್ಕೆ ಮುಂದುವರಿಸಲಾಗಿದ್ದು, ಮೇಲೆ ಓದಲಾದ (4)ರ ಸರ್ಕಾರದ ಆದೇಶ ಮತ್ತು ತಿದ್ದೋಲೆಯಲ್ಲಿ ವಿಶೇಷ ಕೋಶದೊಂದಿಗೆ

ಸದರಿ ಹುದ್ದೆಗಳನ್ನು ದಿನಾಂಕ: 01–04–2008 ರಿಂದ 31–03–2009 ರವರೆಗೆ ಮುಂದುವರಿಸಲಾಗಿದ್ದು, ವಿಶೇಷ ಕೋಶ ಹಾಗೂ ಪೂರಕ ಹುದ್ದೆಗಳ ಮುಂದುವರಿಕೆಯು ದಿನಾಂಕ: 31–03–2009 ಕ್ಕೆ ಅಂತ್ಯಗೊಳ್ಳುವುದರಿಂದ, ಈ ಹುದ್ದೆಗಳನ್ನು ಮುಂದುವರಿಸುವಂತೆ ಮೇಲೆ ಕ್ರಮ ಸಂಖ್ಯೆ (5) ರಲ್ಲಿ ಓದಲಾದ ಕಡತದಲ್ಲಿ ಜಲಸಂಪನ್ಮೂಲ ಇಲಾಖೆಯು ಕೋರಿದೆ.

| ಕ್ರ.ಸಂ | ಹುದ್ದೆಯ ಪದನಾಮ | ಹುದೆಗಳ ಸಂಖ್ಯೆ |
|---|---|---|
| 1. | ವಿಶೇಷಾಧಿಕಾರಿ ಹಾಗೂ ಪದನಿಮಿತ್ತ ಉಪ ಕಾರ್ಯದರ್ಶಿ | 1 ಹುದ್ದೆ |
| 2. | ವಿಶೇಷ ಕರ್ತವ್ಯಾಧಿಕಾರಿ (ಅಧೀನ ಕಾರ್ಯದರ್ಶಿ ಕೇಡರ್) | 1 ಹುದ್ದೆ |
| 3. | ಶಾಖಾಧಿಕಾರಿ | 1 ಹುದ್ದೆ |
| 4. | ಹಿರಿಯ ಸಹಾಯಕ | 2 ಹುದ್ದೆ |
| 5. | ಸಹಾಯಕ | 1 ಹುದ್ದೆ |
| 6. | ಶೀಘ್ರಲಿಪಿಗಾರರು | 1 ಹುದ್ದೆ |
| 7. | ಬೆರಳಚ್ಚುಗಾರರು | 1 ಹುದ್ದೆ |
| 8.. | ದಲಾಯತ್ | 1 ಹುದ್ದೆ |

**ವಿಶೇಷಾಧಿಕಾರಿ ಮತ್ತು ಪದನಿಮಿತ್ತ ಉಪ ಕಾರ್ಯದರ್ಶಿ ಆಪ್ತ ಶಾಖೆ ಸಿಬ್ಬಂದಿ:–**

| ಕ್ರ.ಸಂ | ಹುದ್ದೆಯ ಪದನಾಮ | ಹುದೆಗಳ ಸಂಖ್ಯೆ |
|---|---|---|
| 1. | ಶೀಘ್ರಲಿಪಿಗಾರರು | 1 ಹುದ್ದೆ |
| 2. | ಕಿರಿಯ ಸಹಾಯಕರು | 1 ಹುದ್ದೆ |
| 3. | ಗ್ರೂಪ್–ಡಿ | 1 ಹುದ್ದೆ |

ಪ್ರಸ್ತಾವನೆಯನ್ನು ಪರಿಶೀಲಿಸಿದ ಸರ್ಕಾರವು ಈ ಮುಂದಿನಂತೆ ಆದೇಶಿಸುತ್ತದೆ.

**ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 233 ಸಅಸೇ 2009, ಬೆಂಗಳೂರು, ದಿನಾಂಕ: 15ನೇ ಮೇ 2009**

ಕರ್ನಾಟಕ ಸರ್ಕಾರದ ಸಚಿವಾಲಯದ ಜಲಸಂಪನ್ಮೂಲ ಇಲಾಖೆಯಲ್ಲಿ ಕೃಷ್ಣಾ ಭಾಗ್ಯ ಜಲ ನಿಗಮದ ವಿಶೇಷ ಕೋಶವನ್ನು ಹಾಗೂ ಈ ಕೆಳಕಂಡ ತಾತ್ಕಾಲಿಕ ಹುದ್ದೆಗಳೊಂದಿಗೆ ದಿನಾಂಕ: 01–04–2009 ರಿಂದ ದಿನಾಂಕ: 31–03–2010 ರವರೆಗೆ ಮುಂದುವರಿಸಿ ಆದೇಶಿಸಿದೆ.

| ಕ್ರ.ಸಂ | ಹುದ್ದೆಯ ಪದನಾಮ | ಹುದೆಗಳ ಸಂಖ್ಯೆ |
|---|---|---|
| 1. | ವಿಶೇಷಾಧಿಕಾರಿ ಹಾಗೂ ಪದನಿಮಿತ್ತ ಉಪ ಕಾರ್ಯದರ್ಶಿ | 1 ಹುದ್ದೆ |
| 2. | ವಿಶೇಷ ಕರ್ತವ್ಯಾಧಿಕಾರಿ (ಅಧೀನ ಕಾರ್ಯದರ್ಶಿ ಕೇಡರ್) | 1 ಹುದ್ದೆ |
| 3. | ಶಾಖಾಧಿಕಾರಿ | 1 ಹುದ್ದೆ |
| 4. | ಹಿರಿಯ ಸಹಾಯಕ | 2 ಹುದ್ದೆ |
| 5. | ಸಹಾಯಕ | 1 ಹುದ್ದೆ |
| 6. | ಶೀಘ್ರಲಿಪಿಗಾರರು | 1 ಹುದ್ದೆ |
| 7. | ಬೆರಳಚ್ಚುಗಾರರು | 1 ಹುದ್ದೆ |
| 8.. | ದಲಾಯತ್ | 1 ಹುದ್ದೆ |

**ವಿಶೇಷಾಧಿಕಾರಿ ಮತ್ತು ಪದನಿಮಿತ್ತ ಉಪ ಕಾರ್ಯದರ್ಶಿ ಆಪ್ತ ಶಾಖೆ ಸಿಬ್ಬಂದಿ:–**

| ಕ್ರ.ಸಂ | ಹುದ್ದೆಯ ಪದನಾಮ | ಹುದೆಗಳ ಸಂಖ್ಯೆ |
|---|---|---|
| 1. | ಶೀಘ್ರಲಿಪಿಗಾರರು | 1 ಹುದ್ದೆ |
| 2. | ಕಿರಿಯ ಸಹಾಯಕರು | 1 ಹುದ್ದೆ |
| 3. | ಗ್ರೂಪ್–ಡಿ | 1 ಹುದ್ದೆ |

ಈ ಆದೇಶವನ್ನು ಸರ್ಕಾರದ ಆದೇಶ ಸಂಖ್ಯೆ: ಎಫ್.ಡಿ 1 ಟಿಎಫ್‌ಪಿ 96, ದಿನಾಂಕ: 10–07–1996 ರಲ್ಲಿ ಪ್ರತ್ಯಾಯೋಜಿಸಿರುವ ಅಧಿಕಾರದ ಅನ್ವಯ ಆರ್ಥಿಕ ಇಲಾಖೆ ಸಹಮತಿ ನೀಡಿದೆ ಎಂದು ಪರಿಭಾವಿಸಿ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎಂ.ಎಸ್. ಶಿವರಾಮ್**

ಪಿ.ಆರ್. 1382

ಸರ್ಕಾರದ ಅಧೀನ ಕಾರ್ಯದರ್ಶಿ,
ಸಿಬ್ಬಂದಿ ಮತ್ತು ಆಡಳಿತ ಸುಧಾರಣಾ ಇಲಾಖೆ (ಸೇವೆಗಳು–3).

**ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 06 ಇಮುವಿ 2009, ಬೆಂಗಳೂರು, ದಿನಾಂಕ: 5ನೇ ಜೂನ್ 2009**

**ವಿಷಯ:** ಶ್ರೀ ಎಸ್. ಸಿ. ಜಯಚಂದ್ರ, ಮುಖ್ಯ ಇಂಜಿನಿಯರ್ ಅವರ ವಿರುದ್ಧ ಲೋಕಾಯುಕ್ತ ತನಿಖೆಯನ್ನು ಕಾಯ್ದಿಟ್ಟು ಅವರನ್ನು ಸೇವೆಯಿಂದ ಅಮಾನತ್ತಿನಲ್ಲಿಡುವ ಬಗ್ಗೆ.

ಶ್ರೀ ಎಸ್. ಸಿ. ಜಯಚಂದ್ರ, ಮುಖ್ಯ ಇಂಜಿನಿಯರ್, ಹೇಮಾವತಿ ಯೋಜನೆ, ಗೊರೂರು, ಹಾಸನ ಜಿಲ್ಲೆ, ಅವರು ಅವರ ಸೇವಾವಧಿಯಲ್ಲಿ ಬಲ್ಲ ಆದಾಯದ ಮೂಲಗಳಿಗಿಂತ ಅಪಾರ ಪ್ರಮಾಣದಲ್ಲಿ ಸ್ಥಿರಾಸಿ–ಚರಾಸ್ತಿಗಳನ್ನು ಹೊಂದಿರುವುದು ಕರ್ನಾಟಕ ಲೋಕಾಯುಕ್ತದ ಪೋಲಿಸರು, ಅವರ ಮನೆಯನ್ನು ಶೋಧಿಸಿದಾಗ ಕಂಡು ಬಂದಿರುವುದರಿಂದಲೂ,

ಶ್ರೀ ಎಸ್. ಸಿ. ಜಯಚಂದ್ರ ಅವರ ಮನೆ ಶೋಧನೆಯ ಸಮಯದಲ್ಲಿ ಅಪಾರ ಪ್ರಮಾಣದ ಸ್ಥಿರ ಮತ್ತು ಚರಾಸ್ತಿಗಳು, ನಿವೇಶನ, ಚಿನ್ನ, ಬೆಳ್ಳಿ, ನಗದು, ಬ್ಯಾಂಕ್ ಶಿಲ್ಕು, ವಾಹನಗಳು, ಎಲೆಕ್ಟ್ರಿಕಲ್ ಮತ್ತು ಎಲೆಕ್ಟ್ರಾನಿಕ್ ವಸ್ತುಗಳು, ಬೆಲೆಬಾಳುವ ಪೀಠೋಪಕರಣಗಳು, ಗೃಹೋಪಯೋಗಿ ವಸ್ತುಗಳು ಮತ್ತು ದಾಖಲೆಗಳು ಪತ್ತೆಯಾಗಿರುವುದರಿಂದಲೂ,

ಮೇಲ್ಕಂಡ ಅಕ್ರಮಗಳಿಗಾಗಿ ಶ್ರೀ ಎಸ್. ಸಿ. ಜಯಚಂದ್ರ, ಮುಖ್ಯ ಇಂಜಿನಿಯರ್, ಅವರ ವಿರುದ್ಧ ಲೋಕಾಯುಕ್ತ ತನಿಖೆಯನ್ನು ಕಾಯ್ದಿಟ್ಟು ಅವರನ್ನು ಸೇವೆಯಿಂದ ಅಮಾನತ್ತುಗೊಳಿಸುವುದು ಅವಶ್ಯವೆಂದು ಕಂಡುಬಂದಿರುವುದರಿಂದಲೂ,

ಆದ್ದರಿಂದ ಕರ್ನಾಟಕ ನಾಗರೀಕ ಸೇವಾ (ವರ್ಗೀಕರಣ, ನಿಯಂತ್ರಣ ಮತ್ತು ಮೇಲ್ಮನವಿ) ನಿಯಾಮವಳಿ 1957 ರ ನಿಯಮ 10(1)(ಅಅ) ರಲ್ಲಿ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ ಸರ್ಕಾರವು ಶ್ರೀ ಎಸ್. ಸಿ. ಜಯಚಂದ್ರ, ಮುಖ್ಯ ಇಂಜಿನಿಯರ್, ಹೇಮಾವತಿ ಯೋಜನೆ ಗೊರೂರು, ಹಾಸನ ಜಿಲ್ಲೆ ಅವರನ್ನು ಅವರ ವಿರುದ್ಧ ಮೇಲೆ ಹೇಳಿದ ಆರೋಪಗಳಿಗಾಗಿ ಲೋಕಾಯುಕ್ತ ತನಿಖೆಯನ್ನು ಕಾಯ್ದಿಟ್ಟು ತಕ್ಷಣದಿಂದ ಜಾರಿಗೆ ಬರುವಂತೆ ಹಾಗೂ ಮುಂದಿನ ಆದೇಶದವರೆಗೆ ಈ ಮೂಲಕ ಸೇವೆಯಿಂದ ಅಮಾನತ್ತಿನಲ್ಲಿಡುತ್ತದೆ.

ಅಮಾನತ್ತಿನ ಅವಧಿಯಲ್ಲಿ ಶ್ರೀ ಎಸ್. ಸಿ. ಜಯಚಂದ್ರ, ಮುಖ್ಯ ಇಂಜಿನಿಯರ್, ಅವರು ಕರ್ನಾಟಕ ನಾಗರೀಕ ಸೇವಾ ನಿಯಮಗಳ 98 ನೇ ನಿಯಮದ ಅನ್ವಯ ಜೀವನಾಧಾರ ಭತ್ಯೆಯನ್ನು ಪಡೆಯುತ್ತಾರೆ.

ಅಮಾನತ್ತಿನ ಅವಧಿಯಲ್ಲಿ ಶ್ರೀ ಎಸ್. ಸಿ. ಜಯಚಂದ್ರ, ಮುಖ್ಯ ಇಂಜಿನಿಯರ್, ಅವರು ಸಕ್ಷಮ ಪ್ರಾಧಿಕಾರ ಅನುಮೋದನೆ ಪಡೆಯದೆ ತಾವು ಕಾರ್ಯ ನಿರ್ವಹಿಸುತ್ತಿರುವ ಕೇಂದ್ರ ಸ್ಥಾನವನ್ನು ಬಿಡತಕ್ಕದ್ದಲ್ಲ.

ಶ್ರೀ ಎಸ್. ಸಿ. ಜಯಚಂದ್ರ, ಮುಖ್ಯ ಇಂಜಿನಿಯರ್, ಅವರ ಸ್ಥಾನದಲ್ಲಿ ತಾತ್ಕಾಲಿಕವಾಗಿ ಬದಲಿ ವ್ಯವಸ್ಥೆಯನ್ನು ಮಾಡಲು ಸರ್ಕಾರದ ಪ್ರಧಾನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ, ಅವರು ಕ್ರಮ ಕೈಗೊಳ್ಳುತ್ತಾರೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎಂ.ಎಸ್. ಶಿವರಾಮ್**

ಪಿ.ಆರ್. 1476

ಸರ್ಕಾರದ ಅಧೀನ ಕಾರ್ಯದರ್ಶಿ,
ಸಿಬ್ಬಂದಿ ಮತ್ತು ಆಡಳಿತ ಸುಧಾರಣಾ ಇಲಾಖೆ (ಸೇವೆಗಳು–3).

**ವಿಷಯ:** ಕರ್ನಾಟಕ ಸರ್ಕಾರ ಸಚಿವಾಲಯದ ಅರಣ್ಯ, ಪರಿಸರ ಮತ್ತು ಜೀವಿ ಶಾಸ್ತ್ರ ಇಲಾಖೆಯ ಸರ್ಕಾರದ ಕಾರ್ಯದರ್ಶಿ(ಪರಿಸರ ಮತ್ತು ಜೀವಿಶಾಸ್ತ್ರ) ಹುದ್ದೆಯನ್ನು ಮುಂದುವರಿಸುವ ಬಗ್ಗೆ.

**ಓದಲಾಗಿದೆ:**
1 ಸರ್ಕಾರಿ ಆದೇಶ ಸಂಖ್ಯೆ: ಡಿಪಿಎಆರ್ 464 ಎಸ್ ಎ ಎಸ್ 1998, ದಿನಾಂಕ: 14–07–1999.
2 ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 227 ಸಸಿವಿ 2007, ದಿನಾಂಕ: 28–04–2007.
3 ಅನಧಿಕೃತ ಟಿಪ್ಪಣಿ ಸಂಖ್ಯೆ: ಅಪಜೀ 37 ಇಪಿಸಿ 2003, ದಿನಾಂಕ: 25–04–2009.

**ಪ್ರಸ್ತಾವನೆ:–**

ಕರ್ನಾಟಕ ಸರ್ಕಾರದ ಸಚಿವಾಲಯದ ಅರಣ್ಯ, ಪರಿಸರ ಮತ್ತು ಜೀವಿಶಾಸ್ತ್ರ ಇಲಾಖೆಯ ಸರ್ಕಾರದ ಕಾರ್ಯದರ್ಶಿ (ಪರಿಸರ ಮತ್ತು ಜೀವಿಶಾಸ್ತ್ರ) ಹುದ್ದೆಯನ್ನು ತಾತ್ಕಾಲಿಕವಾಗಿ ಸೃಜಿಸಿ ಕಾಲಕಾಲಕ್ಕೆ ಮುಂದುವರಿಸಲಾಗಿದೆ. ಮೇಲೆ ಕ್ರಮ ಸಂಖ್ಯೆ (2) ರಲ್ಲಿ ಓದಲಾದ ದಿನಾಂಕ: 28–04–2007 ರ ಆದೇಶದಲ್ಲಿ ಈ ಹುದ್ದೆಯನ್ನು ದಿನಾಂಕ:01.04.2007 ರಿಂದ 31–03–2008 ರವರೆಗೆ ಮುಂದುವರಿಸಲಾಗಿದೆ.

ಮೇಲೆ ಕ್ರಮ ಸಂಖ್ಯೆ (3) ರಲ್ಲಿ ಓದಲಾದ ಅನಧಿಕೃತ ಟಿಪ್ಪಣಿಯಲ್ಲಿ ಸರ್ಕಾರದ ಕಾರ್ಯದರ್ಶಿ (ಪರಿಸರ ಮತ್ತು ಜೀವಿಶಾಸ್ತ್ರ) ಹುದ್ದೆಯನ್ನು ದಿನಾಂಕ: 01–04–2007 ರಿಂದ 31–03–2010 ರವರೆಗೆ ಮುಂದುವರಿಸುವಂತೆ ಕೋರಲಾಗಿದೆ.

ಪ್ರಸ್ತಾವನೆಯನ್ನು ಪರಿಶೀಲಿಸಿದ ಸರ್ಕಾರವು ಈ ಮುಂದಿನಂತೆ ಆದೇಶಿಸುತ್ತದೆ.

**ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 276 ಸಅಸೇ 2009, ಬೆಂಗಳೂರು, ದಿನಾಂಕ: 05ನೇ ಜೂನ್ 2009**

ಕರ್ನಾಟಕ ಸರ್ಕಾರದ ಸಚಿವಾಲಯದ ಅರಣ್ಯ, ಪರಿಸರ ಮತ್ತು ಜೀವಿಶಾಸ್ತ್ರ ಇಲಾಖೆಯ ಸರ್ಕಾರದ ಕಾರ್ಯದರ್ಶಿ (ಪರಿಸರ ಮತ್ತು ಜೀವಿಶಾಸ್ತ್ರ) ಹುದ್ದೆಯನ್ನು ದಿನಾಂಕ: 01–04–2008 ರಿಂದ 31–03–2010 ರವರೆಗೆ ತಾತ್ಕಾಲಿಕವಾಗಿ ಮುಂದುವರಿಸಿ ಆದೇಶಿಸಿದೆ.

ಈ ಆದೇಶವನ್ನು ಸರ್ಕಾರದ ಆದೇಶ ಸಂಖ್ಯೆ: ಎಫ್.ಡಿ 1 ಟಿಎಫ್‌ಪಿ 96, ದಿನಾಂಕ: 10–07–1996 ರಲ್ಲಿ ಪ್ರತ್ಯಾಯೋಜಿಸಿರುವ ಅಧಿಕಾರದ ಅನ್ವಯ ಆರ್ಥಿಕ ಇಲಾಖೆ ಸಹಮತಿ ನೀಡಿದೆ ಎಂದು ಪರಿಭಾವಿಸಿ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎಂ.ಎಸ್. ಶಿವರಾಮ್**

ಪಿ.ಆರ್. 1477 ಸರ್ಕಾರದ ಅಧೀನ ಕಾರ್ಯದರ್ಶಿ,

ಸಿಬ್ಬಂದಿ ಮತ್ತು ಆಡಳಿತ ಸುಧಾರಣಾ ಇಲಾಖೆ (ಸೇವೆಗಳು–3).

**ವಿಷಯ:** ಕರ್ನಾಟಕ ಸರ್ಕಾರ ಸಚಿವಾಲಯದ ಲೋಕೋಪಯೋಗಿ ಇಲಾಖೆಯ ವ್ಯಾಪ್ತಿಯಲ್ಲಿರುವ ಬೆಂಗಳೂರು–ಮೈಸೂರು ಇನ್‌ಫ್ರಾಸ್ಟ್ರಕ್ಚರ್ ಕಾರಿಡಾರ್ ಯೋಜನೆ ಶಾಖೆಯಲ್ಲಿನ ಉಪಕಾರ್ಯದರ್ಶಿ (ಕಾನೂನು) ಮತ್ತು ಕಾರ್ಯಪಾಲಕ ಇಂಜಿನಿಯರ್ ಹುದ್ದೆಗಳನ್ನು ರದ್ದುಪಡಿಸುವ ಬಗ್ಗೆ.

**ಓದಲಾಗಿದೆ:** 1) ಸರ್ಕಾರಿ ಆದೇಶ ಸಂಖ್ಯೆ ಸಿಆಸುಇ 148 ಸಅಸೇ 08 ದಿನಾಂಕ 3–12–2008.

2) ಅನಧಿಕೃತ ಟಿಪ್ಪಣಿ ಸಂಖ್ಯೆಃ ಲೋಇ 5 ಸಿಆರ್‌ಎಂ 08 ದಿನಾಂಕ 7–2–2009.

**ಪ್ರಸ್ತಾವನೆ:**

ಮೇಲೆ (1)ರಲ್ಲಿ ಓದಲಾದ ದಿನಾಂಕ 3–12–2008ರ ಸರ್ಕಾರಿ ಆದೇಶದಲ್ಲಿ ಸಚಿವಾಲಯದ ಲೋಕೋಪಯೋಗಿ ಇಲಾಖೆಯಲ್ಲಿನ ಬೆಂಗಳೂರು–ಮೈಸೂರು ಇನ್‌ಫ್ರಾಸ್ಟ್ರಕ್ಚರ್ ಕಾರಿಡಾರ್ ಶಾಖೆಯಲ್ಲಿದ್ದ ಉಪ ಕಾರ್ಯದರ್ಶಿ (ಕಾನೂನು) ಹಾಗೂ ಕಾರ್ಯಪಾಲಕ ಇಂಜಿನಿಯರ್‌ಗಳ ಪೂರಕ ಸಿಬ್ಬಂದಿ ಹುದ್ದೆಗಳನ್ನು ತಕ್ಷಣದಿಂದ ಜಾರಿಗೆ ಬರುವಂತೆ ರದ್ದುಪಡಿಸಲಾಗಿತ್ತು. ಲೋಕೋಪಯೋಗಿ ಇಲಾಖೆಯು ಮೇಲೆ (2) ರಲ್ಲಿ ಓದಲಾದ ದಿನಾಂಕ 7–2–2009ರ ಅನಧಿಕೃತ ಟಿಪ್ಪಣಿಯಲ್ಲಿ ಉಪ ಕಾರ್ಯದರ್ಶಿ (ಕಾನೂನು) ಈ ಹುದ್ದೆಯನ್ನೂ ಸಹ ರದ್ದುಪಡಿಸುವಂತೆ ಹಾಗೂ ಕಾರ್ಯಪಾಲಕ ಇಂಜಿನಿಯರ್ ಹುದ್ದೆಯಲ್ಲಿ ಶ್ರೀ ಬಸವರಾಜ ಎಂ. ದೊಡ್ಡಮನಿ ಅವರು ಕಾರ್ಯ ನಿರ್ವಹಿಸುತ್ತಿದ್ದು, ಅವರಿಗೆ ವೇತನ ಪಡೆಯಲು ಅನುಕೂಲವಾಗುವಂತೆ ಸದರಿ ಹುದ್ದೆಯನ್ನು ದಿನಾಂಕ 31–3–2009ರವರೆಗೆ ಮುಂದುವರೆಸಿ ನಂತರ ಅದನ್ನು ರದ್ದುಪಡಿಸುವಂತೆ ಕೋರಿದೆ. ಇದನ್ನು ಪರಿಶೀಲಿಸಿ ಈ ಮುಂದಿನಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ ಸಿಆಸುಇ 148 ಸಅಸೇ 2008, ಬೆಂಗಳೂರು, ದಿನಾಂಕ 6ನೇ ಜೂನ್ 2009**.

ಕರ್ನಾಟಕ ಸರ್ಕಾರ ಸಚಿವಾಲಯದ ಲೋಕೋಪಯೋಗಿ ಇಲಾಖೆಯ ಬಿ.ಎಂ.ಐ.ಸಿ.ಪಿ. ಶಾಖೆಯಲ್ಲಿದ್ದ ಉಪಕಾರ್ಯದರ್ಶಿ (ಕಾನೂನು) ಈ ಹುದ್ದೆಯನ್ನು ದಿನಾಂಕ 3–12–2008ರಿಂದಲೇ ಜಾರಿಗೆ ಬರುವಂತೆ ರದ್ದುಪಡಿಸಲಾಗಿದೆ. ಕಾರ್ಯಪಾಲಕ ಇಂಜಿನಿಯರ್ ಹುದ್ದೆಯನ್ನು ದಿನಾಂಕ 31–3–2009ರ ವರೆಗೆ ಮುಂದುವರೆಸಿ ಆನಂತರ ಸದರಿ ಹುದ್ದೆಯನ್ನು ರದ್ದುಪಡಿಸಲಾಗಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಟಿಪ್ಪಣಿ ಸಂಖ್ಯೆಃ ಆಇ 202 ವೆಚ್ಚ–12/2009, ದಿನಾಂಕ 12–5–2009ರಲ್ಲಿ ನೀಡಿದ ಸಹಮತಿ ಮೇರೆಗೆ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎಂ.ಎಸ್. ಶಿವರಾಮ್**

ಪಿ.ಆರ್. 1478 ಸರ್ಕಾರದ ಅಧೀನ ಕಾರ್ಯದರ್ಶಿ,

ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ (ಸೇವೆಗಳು–3)

**ವಿಷಯ:** ಕರ್ನಾಟಕ ಸರ್ಕಾರದ ಸಚಿವಾಲಯದ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆಯ ನಿರ್ದೇಶಕರು(ಸ್ವ–ಉದ್ಯೋಗ ಕಾರ್ಯಕ್ರಮ ಶಾಖೆ) ಹಾಗೂ ಪದನಿಮಿತ್ತ ಉಪ/ಜಂಟಿ ಕಾರ್ಯದರ್ಶಿ ಹುದ್ದೆಯನ್ನು ಮುಂದುವರಿಸುವ ಬಗ್ಗೆ.

**ಓದಲಾಗಿದೆ:** 1 ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 46 ಸಸಿವಿ 2006, ದಿನಾಂಕ: 15–06–2006.

2 ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 744 ಸಅಸೇ 2008, ದಿನಾಂಕ: 11–09–2008.

3 ಸರ್ಕಾರದ ಕಾರ್ಯದರ್ಶಿಗಳು, ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆ ಇವರ ಅನಧಿಕೃತ ಟಿಪ್ಪಣಿ ಸಂಖ್ಯೆ: ಗ್ರಾಅಪ:13 ಎಸ್‌ಜೆಸಿ 07, ದಿನಾಂಕ: 14–05–2009.

**ಪ್ರಸ್ತಾವನೆ:–**

ಕರ್ನಾಟಕ ಸರ್ಕಾರದ ಸಚಿವಾಲಯದ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆಯ ನಿರ್ದೇಶಕರು (ಸ್ವ–ಉದ್ಯೋಗ ಕಾರ್ಯಕ್ರಮ) ಹಾಗೂ ಪದನಿಮಿತ್ತ ಸರ್ಕಾರದ ಜಂಟಿ ಕಾರ್ಯದರ್ಶಿ ಹುದ್ದೆಯನ್ನು ತಾತ್ಕಾಲಿಕವಾಗಿ ಸೃಜಿಸಿ ಕಾಲಕಾಲಕ್ಕೆ ಮುಂದುವರಿಸಲಾಗಿದೆ. ಮೇಲೆ ಕ್ರಮ ಸಂಖ್ಯೆ (2) ರಲ್ಲಿ ಓದಲಾದ ದಿನಾಂಕ: 11–09–2008 ರ ಆದೇಶದಲ್ಲಿ ಈ ಹುದ್ದೆಯನ್ನು ದಿನಾಂಕ: 25–06–2009 ರಿಂದ 24–06–2009 ರವರೆಗೆ ಮುಂದುವರಿಸಲಾಗಿದೆ.

ಮೇಲೆ ಕ್ರಮಸಂಖ್ಯೆ(3) ರಲ್ಲಿ ಓದಲಾದ ಅನಧಿಕೃತ ಟಿಪ್ಪಣಿಯಲ್ಲಿ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆಯ ನಿರ್ದೇಶಕರು (ಸ್ವ–ಉದ್ಯೋಗ ಕಾರ್ಯಕ್ರಮ) ಹಾಗೂ ಸರ್ಕಾರದ ಉಪ/ಜಂಟಿ ಕಾರ್ಯದರ್ಶಿ ಹುದ್ದೆಯನ್ನು ದಿನಾಂಕ: 25–06–2009 ರಿಂದ ಒಂದು ವರ್ಷದ ಅವಧಿ ಮುಂದುವರಿಸುವಂತೆ ಕೋರಲಾಗಿದೆ.

ಪ್ರಸ್ತಾವನೆಯನ್ನು ಪರಿಶೀಲಿಸಿದ ಸರ್ಕಾರವು ಈ ಮುಂದಿನಂತೆ ಆದೇಶಿಸುತ್ತದೆ.

**ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 302 ಸಅಸೇ 2009, ಬೆಂಗಳೂರು, ದಿನಾಂಕ: 9ನೇ ಜೂನ್ 2009**

ಕರ್ನಾಟಕ ಸರ್ಕಾರದ ಸಚಿವಾಲಯದ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆಯ ನಿರ್ದೇಶಕರು (ಸ್ವ–ಉದ್ಯೋಗ ಕಾರ್ಯಕ್ರಮ) ಹಾಗೂ ಪದನಿಮಿತ್ತ ಸರ್ಕಾರದ ಉಪ/ಜಂಟಿ ಕಾರ್ಯದರ್ಶಿ ಹುದ್ದೆಯನ್ನು ದಿನಾಂಕ: 25–06–2009 ರಿಂದ 24–06–2010 ರವರೆಗೆ ತಾತ್ಕಾಲಿಕವಾಗಿ ಮುಂದುವರೆಸಿ ಆದೇಶಿಸಿದೆ.

ಈ ಆದೇಶವನ್ನು ಸರ್ಕಾರದ ಆದೇಶ ಸಂಖ್ಯೆ: ಎಫ್‌ಡಿ 1 ಟಿಎಫ್‌ಪಿ 1996, ದಿನಾಂಕ: 10–07–1996 ರಲ್ಲಿ ಪ್ರತ್ಯಾಯೋಜಿಸಿರುವ ಅಧಿಕಾರದ ಅನ್ವಯ ಆರ್ಥಿಕ ಇಲಾಖೆ ಸಹಮತಿ ನೀಡಿದೆ ಎಂದು ಪರಿಭಾವಿಸಿ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎಂ.ಎಸ್. ಶಿವರಾಮ್**

ಪಿ.ಆರ್. 1479 ಸರ್ಕಾರದ ಅಧೀನ ಕಾರ್ಯದರ್ಶಿ,

ಸಿಬ್ಬಂದಿ ಮತ್ತು ಆಡಳಿತ ಸುಧಾರಣಾ ಇಲಾಖೆ (ಸೇವೆಗಳು–3).

**ವಿಷಯ:** ಯೋಜನಾ ಇಲಾಖೆಯ ಅಪರ/ಜಂಟಿ ಕಾರ್ಯದರ್ಶಿಗಳ ಹುದ್ದೆಯನ್ನು ಪೂರಕ ಸಿಬ್ಬಂದಿ ಹುದ್ದೆಗಳೊಂದಿಗೆ ಮುಂದುವರಿಸುವ ಬಗ್ಗೆ.

**ಓದಲಾಗಿದೆ:** 1 ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 29 ಸಅಸೇ 2008, ದಿನಾಂಕ: 27–02–2008.

2 ಸರ್ಕಾರದ ಅಧಿಸೂಚನೆ ಸಂಖ್ಯೆ: ಸಿಆಸುಇ 220 ಅಸೇವ 2008, ದಿನಾಂಕ: 18–11–2008.

3 ಯೋಜನಾ ಇಲಾಖೆಯ ಕಡತ ಸಂಖ್ಯೆ: ಪಿಡಿಎಸ್ 8 ಎಸ್‌ಪಿಬಿ/ಹೆಚ್‌ಪಿಸಿ 2009.

**ಪ್ರಸ್ತಾವನೆ:–**

ಮೇಲೆ ಕ್ರಮ ಸಂಖ್ಯೆ (1) ರಲ್ಲಿ ಓದಲಾದ ದಿನಾಂಕ: 27–02–2008 ರ ಸರ್ಕಾರಿ ಆದೇಶದಲ್ಲಿ ಯೋಜನಾ ಇಲಾಖೆಯ ಸರ್ಕಾರದ ಅಪರ ಕಾರ್ಯದರ್ಶಿ ಹುದ್ದೆಯನ್ನು ಪೂರಕ ಹುದ್ದೆಗಳೊಂದಿಗೆ ಸೃಜಿಸಿ ದಿನಾಂಕ:30–03–2009 ರವರೆಗೆ ಮುಂದುವರಿಸಲಾಗಿದೆ. ಮೇಲೆ ಕ್ರಮಸಂಖ್ಯೆ (2) ರ ಅಧಿಸೂಚನೆ ದಿನಾಂಕ:18–11–2008 ರಲ್ಲಿ ಯೋಜನಾ ಇಲಾಖೆಯ ಅಪರ ಕಾರ್ಯದರ್ಶಿ ಹುದ್ದೆಗೆ ಜಂಟಿ ಕಾರ್ಯದರ್ಶಿಯವರನ್ನು ನೇಮಿಸಲಾಗಿದೆ. ಮೇಲೆ ಕ್ರಮ ಸಂಖ್ಯೆ (3) ರಲ್ಲಿ ಓದಲಾದ ಕಡತದಲ್ಲಿ ಯೋಜನಾ ಇಲಾಖೆಯು ದಿನಾಂಕ: 27–02–2008 ರ ಆದೇಶದಲ್ಲಿ ಸೃಜಿಸಲಾದ ಹುದೆಗಳನ್ನು ದಿನಾಂಕ: 30–03–2009 ರಿಂದ 1 ವರ್ಷಕ್ಕೆ ಮುಂದುವರಿಸುವಂತೆ ಕೋರಲಾಗಿದೆ. ಪ್ರಸ್ತಾವನೆಯನ್ನು ಪರಿಶೀಲಿಸಿದ ಸರ್ಕಾರವು ಈ ಮುಂದಿನಂತೆ ಆದೇಶಿಸುತ್ತದೆ.

**ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 290 ಸಅಸೇ 2009, ಬೆಂಗಳೂರು, ದಿನಾಂಕ: 10ನೇ ಜೂನ್ 2009**.

ಯೋಜನಾ ಇಲಾಖೆಯಲ್ಲಿಯ ಜಂಟಿ ಕಾರ್ಯದರ್ಶಿ/ಅಪರ ಕಾರ್ಯದರ್ಶಿಗಳ ಹುದ್ದೆಯನ್ನು ದಿನಾಂಕ: 31–03–2009 ರಿಂದ ಜಾರಿಗೆ ಬರುವಂತೆ ಹಾಗೂ ಒಂದು ವರ್ಷದ ಅವಧಿಗೆ ಕೆಳಕಂಡ ಪೂರಕ ಸಿಬ್ಬಂದಿ ಹುದ್ದೆಗಳೊಡನೆ ಮುಂದುವರಿಸಲಾಗಿದೆ.

| ಕ್ರಮ ಸಂಖ್ಯೆ | ಹುದ್ದೆಯ ಪದನಾಮ | ಹುದ್ದೆಗಳ ಸಂಖ್ಯೆ |
|---|---|---|
| 1. | ಶೀಘ್ರಲಿಪಿಗಾರ | 1 ಹುದ್ದೆ |
| 2. | ಕಿರಿಯ ಸಹಾಯಕ | 1 ಹುದ್ದೆ |
| 3. | ದಲಾಯತ್/ಜಮೇದಾರ್ | 1 ಹುದ್ದೆ ಹೊರ ಗುತ್ತಿಗೆಯಿಂದ |

ಈ ಆದೇಶವನ್ನು ಸರ್ಕಾರದ ಆದೇಶ ಸಂಖ್ಯೆ: ಎಫ್‌ಡಿ 1 ಟಿಎಫ್‌ಪಿ 1996, ದಿನಾಂಕ: 10–07–1996 ರಲ್ಲಿ ಪ್ರತ್ಯಾಯೋಜಿಸಿರುವ ಅಧಿಕಾರದ ಅನ್ವಯ ಆರ್ಥಿಕ ಇಲಾಖೆ ಸಹಮತಿ ನೀಡಿದೆ ಎಂದು ಪರಿಭಾವಿಸಿ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎಂ.ಎಸ್. ಶಿವರಾಮ್**

ಪಿ.ಆರ್. 1480 ಸರ್ಕಾರದ ಅಧೀನ ಕಾರ್ಯದರ್ಶಿ,

ಸಿಬ್ಬಂದಿ ಮತ್ತು ಆಡಳಿತ ಸುಧಾರಣಾ ಇಲಾಖೆ (ಸೇವೆಗಳು–3).

**ಸಿಬ್ಬಂದಿ ಮತ್ತು ಆಡಳಿತ ಸುಧಾರಣಾ ಸಚಿವಾಲಯ**

**ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 12 ಸೇಇವಿ 2009, ಬೆಂಗಳೂರು, ದಿನಾಂಕ: 11ನೇ ಜೂನ್ 2009**

**ವಿಷಯ:** ಶ್ರೀ ಕೆ.ಸುಬ್ಬಯ್ಯ ಸರ್ಕಾರದ ಅಧೀನ ಕಾರ್ಯದರ್ಶಿ, ಸಮಾಜ ಕಲ್ಯಾಣ ಇಲಾಖೆ, ಕರ್ನಾಟಕ ಸರ್ಕಾರದ ಸಚಿವಾಲಯ ಅವರನ್ನು ಸೇವೆಯಿಂದ ಅಮಾನತ್ತಿನಲ್ಲಿಡುವ ಬಗ್ಗೆ.

ಶ್ರೀ ಕೆ. ಸುಬ್ಬಯ್ಯ ಅಧೀನ ಕಾರ್ಯದರ್ಶಿ, ಸಮಾಜ ಕಲ್ಯಾಣ ಇಲಾಖೆ, ಕರ್ನಾಟಕ ಸರ್ಕಾರದ ಸಚಿವಾಲಯ, ಅವರು ರಾಜ್ಯದಲ್ಲಿನ ಹಿಂದುಳಿದ ವರ್ಗಗಳ ವರ್ಗೀಕರಣ ಕುರಿತಂತೆ ಸಂಬಂಧಪಟ್ಟ ಸಂಸ್ಥೆಗೆ ಸರ್ಕಾರದ ತೀರ್ಮಾನದಂತೆ ಹಿಂಬರಹ ನೀಡದೆ ತಪ್ಪಾದ ಹಿಂಬರಹ ನೀಡುವ ಮೂಲಕ ಅನಾವಶ್ಯಕ ಗೊಂದಲ ಉಂಟುಮಾಡಿರುವುದು ಸರ್ಕಾರದ ಗಮನಕ್ಕೆ ಬಂದಿರುವುದರಿಂದಲೂ,

ಈ ಹಿಂಬರಹ (ಸಂಖ್ಯೆ: ಸಕಇ 210 ಬಿಸಿಎ 2008 ದಿನಾಂಕ 06.05.2009) ನೀಡುವಾಗ ಹಿರಿಯ ಅಧಿಕಾರಿಗಳ ಅನುಮೋದನೆ ಪಡೆದಿರುವುದಿಲ್ಲ ಎಂಬ ಅಂಶವು ಸರ್ಕಾರದ ಗಮನಕ್ಕೆ ಬಂದಿರುವುದರಿಂದಲೂ,

ಶ್ರೀ ಕೆ.ಸುಬ್ಬಯ್ಯ ಅಧೀನ ಕಾರ್ಯದರ್ಶಿ, ಅವರ ಮೇಲ್ಕಂಡ ವರ್ತನೆಯು ತೀವ್ರ ದುರ್ನಡತೆ ಆಗಿದ್ದು ಇದಕ್ಕಾಗಿ ಅವರ ವಿರುದ್ಧ ಶಿಸ್ತಿನ ಕ್ರಮ ಜರುಗಿಸಲು ಪ್ರಸ್ತಾಪಿಸಿದ್ದು, ಶಿಸ್ತಿನ ಕ್ರಮ ತೆಗೆದುಕೊಳ್ಳುವುದನ್ನು ಕಾಯ್ದಿಟ್ಟು ಅವರನ್ನು ಸೇವೆಯಿಂದ ಅಮಾನತಿನಲ್ಲಿಡುವುದು ಅವಶ್ಯವೆರಂದು ಕಂಡು ಬಂದಿರುವುದರಿಂದಲೂ,

ಆದ್ದರಿಂದ ಕರ್ನಾಟಕ ನಾಗರೀಕ ಸೇವಾ (ವರ್ಗೀಕರಣ, ನಿಯಂತ್ರಣ ಮತ್ತು ಮೇಲ್ಮನವಿ) ನಿಯಮಾವಳಿ 1957ರ ನಿಯಮ 10(1)(ಡಿ) ರಲ್ಲಿ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ ಸರ್ಕಾರವು ಶ್ರೀ ಕೆ.ಸುಬ್ಬಯ್ಯ ಅಧೀನ ಕಾರ್ಯದರ್ಶಿ, ಕರ್ನಾಟಕ ಸರ್ಕಾರದ ಸಚಿವಾಲಯ ಅವರನ್ನು ಅವರ ವಿರುದ್ಧ ಮೇಲೆ ಹೇಳಿದ ಆರೋಪಗಳಿಗಾಗಿ ಶಿಸ್ತಿನ ಕ್ರಮ ಕೈಗೊಳ್ಳುವುದನ್ನು ಕಾಯ್ದಿಟ್ಟು ತಕ್ಷಣದಿಂದ ಜಾರಿಗೆ ಬರುವಂತೆ ಹಾಗೂ ಮುಂದಿನ ಆದೇಶದವರೆಗೆ ಈ ಮೂಲಕ ಸೇವೆಯಿಂದ ಅಮಾನತ್ತಿನಲ್ಲಿಡುತ್ತದೆ.

ಅಮಾನತ್ತಿನ ಅವಧಿಯಲ್ಲಿ ಶ್ರೀ ಕೆ.ಸುಬ್ಬಯ್ಯ, ಅಧೀನ ಕಾರ್ಯದರ್ಶಿ, ಅವರು ಕರ್ನಾಟಕ ನಾಗರೀಕ ಸೇವಾ ನಿಯಮಗಳ 98ನೇ ನಿಯಮದ ಅನ್ವಯ ಜೀವನಾಧಾರ ಭತ್ಯೆಯನ್ನು ಪಡೆಯುತ್ತಾರೆ.

ಅಮಾನತ್ತಿನ ಅವಧಿಯಲ್ಲಿ ಶ್ರೀ ಕೆ.ಸುಬ್ಬಯ್ಯ, ಅಧೀನ ಕಾರ್ಯದರ್ಶಿ, ಅವರು ಸಕ್ಷಮ ಪ್ರಾಧಿಕಾರ ಅನುಮೋದನೆ ಪಡೆಯದೆ ತಾವು ಕಾರ್ಯ ನಿರ್ವಹಿಸುತ್ತಿರುವ ಕೇಂದ್ರ ಸ್ಥಾನವನ್ನು ಬಿಡತಕ್ಕದ್ದಲ್ಲ.

ಶ್ರೀ ಕೆ.ಸುಬ್ಬಯ್ಯ, ಅಧೀನ ಕಾರ್ಯದರ್ಶಿ, ಅವರ ಸ್ಥಾನದಲ್ಲಿ ತಾತ್ಕಾಲಿಕವಾಗಿ ಬದಲಿ ವ್ಯವಸ್ಥೆಯನ್ನು ಮಾಡಲು ಸರ್ಕಾರದ ಕಾರ್ಯದರ್ಶಿ, ಸಮಾಜ ಕಲ್ಯಾಣ ಇಲಾಖೆ ಅವರು ಕ್ರಮ ಕೈಗೊಳ್ಳುತ್ತಾರೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎಂ.ಎಸ್. ಶಿವರಾಮ್**

ಪಿ.ಆರ್. 1481

ಸರ್ಕಾರದ ಅಧೀನ ಕಾರ್ಯದರ್ಶಿ,

ಸಿಬ್ಬಂದಿ ಮತ್ತು ಆಡಳಿತ ಸುಧಾರಣಾ ಇಲಾಖೆ (ಸೇವೆಗಳು–3).

**ವಿಷಯ:** ಕರ್ನಾಟಕ ಸರ್ಕಾರ ಸಚಿವಾಲಯದ ಮೂಲ ಸೌಲಭ್ಯ ಅಭಿವೃದ್ಧಿ ಇಲಾಖೆಯ ಜಂಟಿ ಕಾರ್ಯದರ್ಶಿ ಹುದ್ದೆಗೆ ಪೂರಕ ಸಿಬ್ಬಂದಿ ಹುದ್ದೆಗಳನ್ನು ಸೃಜಿಸುವ ಬಗ್ಗೆ.

**ಓದಲಾಗಿದೆ:**
1. ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 874 ಸಅಸೇ 2008, ದಿನಾಂಕ: 07–03–2009.
2. ಅಧಿಸೂಚನೆ ಸಂಖ್ಯೆ: ಸಿಆಸುಇ 874 ಸಅಸೇ 2008, ದಿನಾಂಕ: 07–03–2009.
3. ಮೂಲ ಸೌಲಭ್ಯ ಅಭಿವೃದ್ಧಿ ಇಲಾಖೆಯ ಸರ್ಕಾರದ ಜಂಟಿ ಕಾರ್ಯದರ್ಶಿ ಇವರ ಟಿಪ್ಪಣಿ ಸಂಖ್ಯೆ:ಐಡಿಡಿ/1/ಜಕಾ/2009, ದಿನಾಂಕ: 16–03–2009.

**ಪ್ರಸ್ತಾವನೆ:–**

ಮೇಲೆ ಕ್ರಮ ಸಂಖ್ಯೆ (1) ರಲ್ಲಿ ಓದಲಾದ ದಿನಾಂಕ: 07–03–2009 ರ ಆದೇಶದಲ್ಲಿ ಮೂಲ ಸೌಲಭ್ಯ ಅಭಿವೃದ್ಧಿ ಇಲಾಖೆಯಲ್ಲಿ ವೇತನ ಶ್ರೇಣಿ ರಹಿತ ಜಂಟಿ ಕಾರ್ಯದರ್ಶಿ ಹುದ್ದೆಯನ್ನು ತಾತ್ಕಾಲಿಕವಾಗಿ ಸೃಜಿಸಲಾಗಿದೆ. ಮೇಲೆ ಕ್ರಮಸಂಖ್ಯೆ (2) ರಲ್ಲಿ ಓದಲಾದ ಅಧಿಸೂಚನೆಯಲ್ಲಿ ಜಂಟಿ ಕಾರ್ಯದರ್ಶಿ ಹುದ್ದೆಗೆ ಶ್ರೀ ಎನ್. ರಮೇಶ್, ಇವರನ್ನು ನೇಮಿಸಲಾಗಿದೆ. ಮೇಲೆ ಕ್ರಮ ಸಂಖ್ಯೆ (3) ರಲ್ಲಿ ಓದಲಾದ ಟಿಪ್ಪಣಿಯಲ್ಲಿ ಜಂಟಿ ಕಾರ್ಯದರ್ಶಿ ಹುದ್ದೆಗೆ ಲಭ್ಯವಿರುವ ಪೂರಕ ಸಿಬ್ಬಂದಿ ಹುದ್ದೆಗಳನ್ನು ಸೃಜಿಸುವಂತೆ ಕೋರಲಾಗಿದೆ. ಈ ಪ್ರಸ್ತಾವನೆಯನ್ನು ಪರಿಶೀಲಿಸಿದ ಸರ್ಕಾರವು ಮುಂದಿನಂತೆ ಆದೇಶಿಸುತ್ತದೆ.

**ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 196 ಸಅಸೇ 2009, ಬೆಂಗಳೂರು, ದಿನಾಂಕ: 19ನೇ ಜೂನ್ 2009.**

ಕರ್ನಾಟಕ ಸರ್ಕಾರ ಸಚಿವಾಲಯದ ಮೂಲ ಸೌಲಭ್ಯ ಅಭಿವೃದ್ಧಿ ಇಲಾಖೆಯಲ್ಲಿ ಸೃಜಿಸಲಾಗಿರುವ ಸರ್ಕಾರದ ಜಂಟಿ ಕಾರ್ಯದರ್ಶಿಯವರ ಆಪ್ತ ಶಾಖೆಗೆ ಈ ಕೆಳಕಂಡ ಹುದ್ದೆಗಳನ್ನು ತಾತ್ಕಲಿಕವಾಗಿ (ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ

874 ಸಅಸೇ 2008, ದಿನಾಂಕ: 07–03–2009 ರಲ್ಲಿ ಸೃಜಿಸಲಾಗಿರುವ ಜಂಟಿ ಕಾರ್ಯದರ್ಶಿ ಹುದ್ದೆ ಅಸ್ತಿತ್ವದಲ್ಲಿರುವವರೆಗೆ) ಸೃಜಿಸಲಾಗಿದೆ.

| ಕ್ರಮ ಸಂಖ್ಯೆ | ಹುದ್ದೆಯ ಪದನಾಮ | ಹುದ್ದೆಗಳ ಸಂಖ್ಯೆ |
|---|---|---|
| 1. | ಶೀಘ್ರಲಿಪಿಗಾರ/ಪತ್ರಾಂಕಿತ ಆಪ್ತ ಸಹಾಯಕರು | 1 ಹುದ್ದೆ |
| 2. | ಕಿರಿಯ ಸಹಾಯಕ | 1 ಹುದ್ದೆ |
| 3. | ದಲಾಯತ್ | 1 ಹುದ್ದೆ |

ಈ ಮೇಲ್ಕಂಡ ಹುದ್ದೆಗಳನ್ನು ಸ್ಥಳಾಂತರಿಸುವ ಮೂಲಕ (By Re-deployment) ಭರ್ತಿ ಮಾಡಲು ಸೂಚಿಸಲಾಗಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಟಿಪ್ಪಣಿ ಸಂಖ್ಯೆ: ಆಇ 496 ವೆಚ್ಚ–12/2009, ದಿನಾಂಕ:01–06–2009 ರಲ್ಲಿ ನೀಡಿರುವ ಸಹಮತಿಯನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎಂ.ಎಸ್. ಶಿವರಾಮ್**

ಪಿ.ಆರ್. 1485 ಸರ್ಕಾರದ ಅಧೀನ ಕಾರ್ಯದರ್ಶಿ,

ಸಿಬ್ಬಂದಿ ಮತ್ತು ಆಡಳಿತ ಸುಧಾರಣಾ ಇಲಾಖೆ (ಸೇವೆಗಳು–3).

**ವಿಷಯ:** ಶ್ರೀ ಹೆಚ್.ಕೆ. ಹೊರ್ತಿಕರ್, ನಿವೃತ್ತ ಮುಖ್ಯ ಇಂಜಿನಿಯರ್, ಅವರ ವಿರುದ್ಧ ಇಲಾಖಾ ವಿಚಾರಣೆ ಬಗ್ಗೆ ಅಂತಿಮ ಆದೇಶ ಕುರಿತು.

**ಓದಲಾಗಿದೆ:** 1) ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 76 ಎಸ್ಇಎನ್ 2005, ದಿನಾಂಕ: 12.09.2006.

2) ಶ್ರೀ ಸೋಸಲೆ ಇಂಧುದರ್, ನಿವೃತ್ತ ನ್ಯಾಯಾಧೀಶರ ಪತ್ರ ದಿನಾಂಕ: 12.05.2009.

**ಪ್ರಸ್ತಾವನೆ:**

ಶ್ರೀ ಹೆಚ್.ಕೆ. ಹೊರ್ತಿಕರ್, ನಿವೃತ್ತ ಮುಖ್ಯ ಇಂಜಿನಿಯರ್ ಅವರು ಮುಖ್ಯ ಇಂಜಿನಿಯರ್ ರಾಷ್ಟ್ರೀಯ ಹೆದ್ದಾರಿ ಬೆಂಗಳೂರು ಇಲ್ಲಿ ಕಾರ್ಯನಿರ್ವಹಿಸುತ್ತಿದ್ದಾಗ ಹೆಗರಿ ಸೇತುವೆ ಸುಂಕ ಸಂಗ್ರಹಣ ಕಾಮಗಾರಿ ಗುತ್ತಿಗೆಯ ಗುತ್ತಿಗೆದಾರರಿಗೆ ಕಡಿಮೆ ದಂಡ ವಿಧಿಸಿ ಕರ್ತವ್ಯ ಲೋಪ ಎಸಗುವ ಮೂಲಕ ಸರ್ಕಾರಕ್ಕೆ ಅಪಾರ ಆರ್ಥಿಕ ನಷ್ಟ ಉಂಟುಮಾಡಿರುವುದು ಹಾಗೂ ಕರಾರಿನಂತೆ ಕ್ರಮ ಜರುಗಿಸದೇ ಕರಾರಿನಲ್ಲಿ ಷರತ್ತನ್ನು ಉದ್ದೇಶ ಪೂರ್ವಕವಾಗಿ ಉಲ್ಲಂಘಿಸಿದ ಆರೋಪಕ್ಕಾಗಿ ಶ್ರೀ ಹೆಚ್.ಕೆ. ಹೊರ್ತಿಕರ್ ನಿವೃತ್ತ ಮುಖ್ಯ ಇಂಜಿನಿಯರ್ ಇವರು ವಿರುದ್ಧ ಕೆ.ಸಿ.ಎಸ್.ಆರ್ ನಿಯಮ 214ರ ರನ್ವಯ ಮೇಲೆ (1)ರಲ್ಲಿ ಓದಲಾದ ದಿನಾಂಕ:12.09.2006 ಸರ್ಕಾರಿ ಆದೇಶದಲ್ಲಿ ಇಲಾಖಾ ವಿಚಾರಣೆಯನ್ನು ಆದೇಶಿಸಿ ನಿವೃತ್ತ ನ್ಯಾಯಾಧೀಶರಾದ ಶ್ರೀ ಎಸ್. ಇಂದೋಧರ ಇವರನ್ನು ವಿಚಾರಣಾಧಿಕಾರಿಯಾಗಿ ನೇಮಿಸಲಾಗಿತ್ತು. ವಿಚಾರಣಾಧಿಕಾರಿಗಳು ಮೇಲೆ (2)ರಲ್ಲಿ ಓದಲಾದ ದಿನಾಂಕ: 12.05.2009ರ ವಿಚಾರಣಾ ವರದಿಯನ್ನು ಸಲ್ಲಿಸಿದ್ದು, ಈ ವಿಚಾರಣಾ ವರದಿಯನ್ನು ಪರಿಶೀಲಿಸಲಾಗಿ, ಈ ಪ್ರಕರಣದ ಸಾಕ್ಷಿದಾರರಾದ ಶ್ರೀ ಮುನಿಕೃಷ್ಣಪ್ಪ, ಕಾರ್ಯಪಾಲಕ ಇಂಜಿನಿಯರ್ ಅವರು ತಮ್ಮ ಲೋಪವನ್ನು ಮುಚ್ಚಿಟ್ಟುಕೊಳ್ಳಲು ಸಲ್ಲಿಸಿದ ಪ್ರಸ್ತಾವನೆಯಿಂದಾಗಿ ಇವರ ವಿರುದ್ಧ ಇಲಾಖಾ ವಿಚಾರಣೆ ಹೂಡಲ್ಪಟ್ಟಿದ್ದು ಶ್ರೀ ಹೆಚ್.ಕೆ. ಹೊರ್ತಿಕರ್ ಇವರಿಂದ ಯಾವುದೇ ಉಲ್ಲಂಘನೆ ಆಗಿಲ್ಲದಿರುವುದು ಮತ್ತು ಅವರು ಅರೆ ನ್ಯಾಯಾಂಗ ಅಧಿಕಾರ (Quasi Judicial Power) ಚಲಾಯಿಸಿ ಕರ್ತವ್ಯ ನಿರ್ವಹಿಸಿರುವುದು ವ್ಯಕ್ತವಾಗಿದೆ. ಆಪಾದಿತರ ಮೇಲೆ ಹೊರಿಸಲಾಗಿರುವ ಆಪಾದನೆಗಳು ರುಜುವಾತಾಗಿರುವುದಿಲ್ಲ ಎಂಬ ವಿಚಾರಣಾಧಿಕಾರಿಗಳ ಅಭಿಪ್ರಾಯವನ್ನು ಒಪ್ಪಿಕೊಂಡು ಸರ್ಕಾರವು ಈ ಮುಂದಿನಂತೆ ಆದೇಶಿಸುತ್ತದೆ.

**ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 76 ಎಸ್ಇಎನ್ 2005, ಬೆಂಗಳೂರು, ದಿನಾಂಕ: 20ನೇ ಜೂನ್ 2009**

ಪ್ರಸ್ತಾವನೆಯಲ್ಲಿ ವಿವರಿಸಲ್ಪಟ್ಟ ಅಂಶಗಳಿಂದಾಗಿ ಸರ್ಕಾರವು ಶ್ರೀ ಹೆಚ್.ಕೆ. ಹೊರ್ತಿಕರ್, ನಿವೃತ್ತ ಮುಖ್ಯ ಇಂಜಿನಿಯರ್, ಅವರನ್ನು ಈ ಪ್ರಕರಣದಲ್ಲಿ ಅವರ ವಿರುದ್ಧ ಮಾಡಲಾದ ಆರೋಪಗಳಿಂದ ಮುಕ್ತರನ್ನಾಗಿಸುತ್ತದೆ.

ಈ ಇಲಾಖಾ ವಿಚಾರಣೆ ನಡೆಯದಿದ್ದಲ್ಲಿ ಶ್ರೀ ಹೆಚ್.ಕೆ. ಹೊರ್ತಿಕರ್ ಇವರು ಯಾವ ಸೌಲಭ್ಯಗಳನ್ನು ಪಡೆಯುತ್ತಿದ್ದರೋ ಅವುಗಳನ್ನು ಪಡೆಯಲು ಅರ್ಹರಾಗಿರುತ್ತಾರೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎಂ.ಎಸ್. ಶಿವರಾಮ್**

ಪಿ.ಆರ್. 1486 ಸರ್ಕಾರದ ಅಧೀನ ಕಾರ್ಯದರ್ಶಿ,

ಸಿಬ್ಬಂದಿ ಮತ್ತು ಆಡಳಿತ ಸುಧಾರಣಾ ಇಲಾಖೆ (ಸೇವೆಗಳು–3).

## ಶಿಕ್ಷಣ ಸಚಿವಾಲಯ

**ವಿಷಯ:** ಸರ್ಕಾರಿ ಜಿಲ್ಲಾ ಮುದ್ರಣಾಲಯ, ಮಂಗಳೂರು, ಇದನ್ನು ತಾತ್ಕಾಲಿಕವಾಗಿ ಬೆಂಗಳೂರಿಗೆ ಸ್ಥಳಾಂತರಿಸುವ ಬಗ್ಗೆ.

**ಓದಲಾಗಿದೆ:** 1) ನಿರ್ದೇಶಕರು, ಮುದ್ರಣ, ಲೇಖನ ಸಾಮಗ್ರಿ ಮತ್ತು ಪ್ರಕಟಣೆಗಳ ಇಲಾಖೆ, ಬೆಂಗಳೂರು, ಇವರ ದಿನಾಂಕ:04/06-11-2008ರ ಪತ್ರ ಸಂಖ್ಯೆ: ಡಿ.ಪಿ.ಎಸ್/ಪಿ.ಎಲ್.ಜಿ-16/2008-09/ಪಿ(ಪಿ)139.

2) ನಿರ್ದೇಶಕರು, ಮುದ್ರಣ, ಲೇಖನ ಸಾಮಗ್ರಿ ಮತ್ತು ಪ್ರಕಟಣೆಗಳ ಇಲಾಖೆ, ಬೆಂಗಳೂರು, ಇವರ ದಿನಾಂಕ:02/11-12-2008ರ ಪತ್ರ ಸಂಖ್ಯೆ: ಡಿ.ಪಿ.ಎಸ್/ಸಿಬ್ಬಂದಿ-ಎ/31/ಪಿ(ಪಿ)1772008-09.

**ಪ್ರಸ್ತಾವನೆ:**

ಮೇಲೆ (1) ರಲ್ಲಿ ಓದಲಾದ ದಿನಾಂಕ:04/06.11.2008ರ ಪತ್ರದನ್ವಯ ನಿರ್ದೇಶಕರು, ಮುದ್ರಣ, ಲೇಖನ ಸಾಮಗ್ರಿ ಮತ್ತು ಪ್ರಕಟಣೆಗಳ ಇಲಾಖೆ, ಬೆಂಗಳೂರು, ಇವರು ಮಂಗಳೂರಿನ ಜಿಲ್ಲಾ ಮುದ್ರಣಾಲಯವನ್ನು 2001ರಲ್ಲಿ, ಯೋಜನೆಯಲ್ಲಿ ಲಭ್ಯವಿರುವ ಹಣದಿಂದ ಪ್ರಾರಂಭಿಸಲಾಗಿರುತ್ತದೆ. ಈ ಮುದ್ರಣಾಲಯದಲ್ಲಿ ಮುದ್ರಿಸಬೇಕಾದ ನಿರ್ದಿಷ್ಟ ಹಾಗೂ ನಿಗದಿತ ಕೆಲಸಗಳು ಇಲ್ಲದಿದ್ದರಿಂದ, ಕೇಂದ್ರ ಮುದ್ರಣಾಲಯದಿಂದಲೇ ಕೆಲಸಗಳನ್ನು ವಹಿಸಿಕೊಡಲಾಗುತ್ತಿತ್ತು. ಇಲ್ಲಿಗೆ ಒಟ್ಟು 51 ವಿವಿಧ ಹುದ್ದೆಗಳು ಮಂಜೂರಾಗಿದ್ದು, ಪ್ರಸ್ತುತ 15 ಹುದ್ದೆಗಳಲ್ಲಿ ಖಾಯಂ ನೌಕರರು ಕಾರ್ಯನಿರ್ವಹಿಸುತ್ತಿರುತ್ತಾರೆ. ಈ ಭಾಗದಲ್ಲಿ ಮುದ್ರಣಕ್ಕೆ ಅಂತಹ ಹೆಚ್ಚುವರಿ ಕೆಲಸಗಳಿರುವುದಿಲ್ಲ. ಹುದ್ದೆಗಳನ್ನು ಭರ್ತಿ ಮಾಡದೆ ಇರುವುದರಿಂದ ಇಲ್ಲಿ ಸೂಕ್ತ ನಿಯಂತ್ರಣ ವ್ಯವಸ್ಥೆಗಳೂ ಸಾಧ್ಯವಿರುವುದಿಲ್ಲ. ಹೀಗಾಗಿ ಇದೊಂದು ಲಾಭದಾಯಕ ಅಥವಾ ಸರ್ಕಾರದ ನಿರ್ದಿಷ್ಟ ಯೋಜನೆಯ ಅನುಷ್ಠಾನಕ್ಕಾಗಲೀ ತೆರೆಯಲಾದ ಮುದ್ರಣಾಲಯವಾಗಿರುವುದಿಲ್ಲ.

2. ಈ ಮುದ್ರಣಾಲಯಕ್ಕೆ ಎರಡು ಕಟ್ಟಡಗಳಿದ್ದು, ಈ ಎರಡು ಕಟ್ಟಡಗಳೂ ಪೂರ್ಣವಾಗಿ ಶಿಥಿಲಗೊಂಡಿದ್ದು, ಇವುಗಳನ್ನು ತಕ್ಷಣ ರಿಪೇರಿ ಮಾಡಿಸುವ ಅವಶ್ಯಕತೆಯಿರುತ್ತದೆ. ಮುಖ್ಯ ಕಟ್ಟಡದಲ್ಲಿರುವ ಕಾಗದ ಉಗ್ರಾಣ ಮಳೆಗೆ ನೆನೆದು, ಒಂದು ಭಾಗವು ಕುಸಿದು ಬಿದ್ದಿರುತ್ತದೆ. ಇನ್ನೊಂದು ಕಟ್ಟಡಕ್ಕೆ ತೀವ್ರ ರೀತಿಯ ರಿಪೇರಿಗಳು ಆಗಬೇಕಿದ್ದು, ಅಲ್ಲಿಯವರೆಗೂ ಇದರ ಬಳಕೆ ಆಗುವುದಿಲ್ಲ. ಈ ಕಟ್ಟಡದ ಗೋಡೆಗಳು ಬೇರೆಯವರ ಶೆಡ್‌ಗಳಿಗೆ ಹೊಂದಿಕೊಂಡಿರುತ್ತವೆ. ಇದರಿಂದ ರಿಪೇರಿ ಕೆಲಸಗಳು ಕಷ್ಟದಾಯಕವಾಗಿರುತ್ತದೆ.

3. ಇಲ್ಲಿ ಪ್ರತಿ ತಿಂಗಳು ಪಾವತಿಸಲಾಗುತ್ತಿರುವ ವೇತನದ ಮೊತ್ತ ಸುಮಾರು 1.66 ಲಕ್ಷ ರೂಪಾಯಿಗಳು. ಇಲ್ಲಿ ಆಗುತ್ತಿರುವ ಉತ್ಪಾದನೆ ಸುಮಾರು 2 ಲಕ್ಷ ಮುದ್ರಣಗಳು ಹಾಗೂ ಸುಮಾರು 2000 ಪುಸ್ತಕಗಳು. ಈಗಿರುವ ಸಿಬ್ಬಂದಿ ಹಾಗೂ ಯಂತ್ರದ ಸ್ಥಿತಿಗತಿಯನ್ನು ಆದರಿಸಿದಲ್ಲಿ ಇಲ್ಲಿ ಇದಕ್ಕಿಂತಲೂ ಹೆಚ್ಚಿನ ಉತ್ಪಾದನೆಯನ್ನು ಪಡೆಯುವ ಸಾಧ್ಯತೆ ಇರುವುದಿಲ್ಲ. ಇಲ್ಲಿ ಹೆಚ್ಚುವರಿ ಉತ್ಪಾದನೆ ಪಡೆಯಬೇಕಾದರೆ ಹೆಚ್ಚಿನ ಸಿಬ್ಬಂದಿಯನ್ನು ನೇಮಿಸಿಕೊಳ್ಳಬೇಕಾಗುತ್ತದೆ. ಹೀಗಾಗಿ ಇಲ್ಲಿನ ಈಗಿನ ಉತ್ಪಾದನೆಯ ಮಾರುಕಟ್ಟೆ ಮೌಲ್ಯ ಸುಮಾರು 15,000 ರೂಪಾಯಿಗಳು ಮಾತ್ರ ಹೀಗಾಗಿ ಇಲ್ಲಿನ ಮುದ್ರಣಾಲಯ ಆರ್ಥಿಕವಾಗಿ ಲಾಭದಾಯಕವಾಗಿಲ್ಲದೆ ಇರುವುದು ಹಾಗೂ ಅಲ್ಲಿನ ಸಿಬ್ಬಂದಿಯ ವೆಚ್ಚವನ್ನಾದರೂ ಸರಿದೂಗಿಸುವಷ್ಟರ ಮಟ್ಟಿಗೆ ಉತ್ಪಾದನೆ ಆಗುತ್ತಿಲ್ಲವೆಂಬ ಅಂಶವೂ ಸಹ ಸ್ಪಷ್ಟವಾಗಿರುತ್ತದೆ.

4. ಈ ಮುದ್ರಣಾಲಯ ವ್ಯವಸ್ಥಿತವಾಗಿ ನಡೆಯಬೇಕಾದರೆ, ಇಲ್ಲಿನ ಕಟ್ಟಡ ಕೂಡಲೇ ರಿಪೇರಿಯಾಗಬೇಕು. ಇಲ್ಲದಿದ್ದಲ್ಲಿ ಇಲ್ಲಿ ಕೆಲಸ ನಿರ್ವಹಿಸುವ ಕೆಲಸಗಾರರಿಗೆ ಅಪಾಯ ಹಾಗೂ ಅಲ್ಲಿನ ಸರ್ಕಾರಿ ವಸ್ತುಗಳಿಗೆ ಸೂಕ್ತ ಭದ್ರತೆ ಇರುವುದಿಲ್ಲ ಹಾಗೂ ಸೂಕ್ತ ಸಿಬ್ಬಂದಿ ನೇಮಕಾತಿ ಆಗಬೇಕಾಗಿರುತ್ತದೆ. ಆದುದರಿಂದ, ಈ ಮುದ್ರಣಾಲಯವನ್ನು ಈ ಹಂತದಲ್ಲಿ ಮುಂದುವರೆಸುವುದು ಸರ್ಕಾರಕ್ಕೆ ಹೊರೆಯಾಗಿರುತ್ತದೆ. ಈ ಎಲ್ಲಾ ಕಾರಣಗಳ ಹಿನ್ನೆಲೆಯಲ್ಲಿ ಸರ್ಕಾರಿ ಜಿಲ್ಲಾ ಮುದ್ರಣಾಲಯ, ಮಂಗಳೂರು, ಇದನ್ನು ಬೆಂಗಳೂರಿಗೆ ವರ್ಗಾಯಿಸುವುದು ಸೂಕ್ತವಾಗಿದ್ದು, ಸದರಿ ಕಟ್ಟಡಗಳನ್ನು ರಿಪೇರಿಗೊಳಿಸಿ ಸಾಕಷ್ಟು ಸಿಬ್ಬಂದಿಯನ್ನು ನೇಮಕಾತಿ ಮಾಡಿದ ನಂತರ ಇದರ ಪುನರಾರಂಭಕ್ಕೆ ಪರಿಶೀಲಿಸಬಹುದಾಗಿದ್ದು, ಅಂತೆಯೇ ಸೂಕ್ತ ಸರ್ಕಾರಿ ಆದೇಶ ಹೊರಡಿಸುವಂತೆ ಕೋರಿ ಪ್ರಸ್ತಾವನೆ ಸಲ್ಲಿಸಿರುತ್ತಾರೆ.

5. ಮೇಲೆ (2)ರಲ್ಲಿ ಓದಲಾದ ದಿನಾಂಕ: 02/11.12.2008ರ ಪತ್ರದನ್ವಯ ನಿರ್ದೇಶಕರು, ಮುದ್ರಣ, ಲೇಖನ ಸಾಮಗ್ರಿ ಮತ್ತು ಪ್ರಕಟಣೆಗಳ ಇಲಾಖೆ, ಬೆಂಗಳೂರು, ಇವರ ಪ್ರಸ್ತಾವನೆಯನ್ನು ಮುಂದುವರೆಸುತ್ತಾ ಸಹಾಯಕ ನಿರ್ದೇಶಕರು, ಸರ್ಕಾರಿ ಜಿಲ್ಲಾ ಮುದ್ರಣಾಲಯ, ಶಿವಮೊಗ್ಗ, ಇವರು ಸರ್ಕಾರಿ ಜಿಲ್ಲಾ ಮುದ್ರಣಾಲಯ, ಶಿವಮೊಗ್ಗ ಇಲ್ಲಿ ಒಂದು ಅಗ್ರಕಾರ್ಮಿಕರ ಹುದ್ದೆ ಖಾಲಿ ಇದ್ದು, ಒಬ್ಬರು ಅಗ್ರಕಾರ್ಮಿಕರ ಅವಶ್ಯಕತೆಯಿರುವುದರಿಂದ ಸರ್ಕಾರಿ ಜಿಲ್ಲಾ ಮುದ್ರಣಾಲಯ, ಮಂಗಳೂರು ಇಲ್ಲಿ ಕಾರ್ಯನಿರ್ವಹಿಸುತ್ತಿರುವ ಶ್ರೀ ಹರೀಶ್, ಅಗ್ರಕಾರ್ಮಿಕರು ಇವರನ್ನು ಖಾಲಿ ಇರುವ ಹುದ್ದೆಗೆ ವರ್ಗಾವಣೆ ಮಾಡುವಂತೆ ಹಾಗೂ ಸದರಿ ಮುದ್ರಣಾಲಯದಲ್ಲಿ ಕಾರ್ಯನಿರ್ವಹಿಸುತ್ತಿರುವ ಶ್ರೀ ಹರಿಕಟ್ಟಿ, ಪ್ರಥಮ ದರ್ಜೆ ಸಹಾಯಕರು,

ಇವರನ್ನು ಹುದ್ದೆ ಸಮೇತ ಸರ್ಕಾರಿ ಜಿಲ್ಲಾ ಮುದ್ರಣಾಲಯ, ಶಿವಮೊಗ್ಗ, ಇಲ್ಲಿಗೆ ಸ್ಥಳಾಂತರಿಸುವಂತೆ ಕೋರಿರುತ್ತಾರೆ. ಸರ್ಕಾರಿ ಜಿಲ್ಲಾ ಮುದ್ರಣಾಲಯ, ಶಿವಮೊಗ್ಗ ಈ ಮುದ್ರಣಾಲಯವು ಉತ್ತಮವಾಗಿ ಕಾರ್ಯನಿರ್ವಹಿಸುತ್ತಿದ್ದು, ಇಲ್ಲಿನ ಸಿಬ್ಬಂದಿ ಕೊರತೆಯನ್ನು ನೀಗಿಸಲು ಸಹಾಯಕ ನಿರ್ದೇಶಕರು, ಸರ್ಕಾರಿ ಜಿಲ್ಲಾ ಮುದ್ರಣಾಲಯ, ಶಿವಮೊಗ್ಗ ಇವರ ಕೋರಿಕೆಯನ್ನು ಪರಿಗಣಿಸಿ, ಸರ್ಕಾರಿ ಜಿಲ್ಲಾ ಮುದ್ರಣಾಲಯ, ಮಂಗಳೂರು, ಇಲ್ಲಿದ್ದ 51 ಮಂಜೂರಾದ ಹುದ್ದೆಗಳಲ್ಲಿ 50 ಹುದ್ದೆಗಳನ್ನು ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು ಇಲ್ಲಿಗೆ ಸ್ಥಳಾಂತರಿಸಿ, ಮತ್ತು ಒಂದು ಹುದ್ದೆಯನ್ನು ಸರ್ಕಾರಿ ಜಿಲ್ಲಾ ಮುದ್ರಣಾಲಯ, ಶಿವಮೊಗ್ಗ, ಇಲ್ಲಿಗೆ ಸ್ಥಳಾಂತರಿಸಿ, ಹುದ್ದೆಯಲ್ಲಿ ಕೆಲಸ ನಿರ್ವಹಿಸುತ್ತಿರುವ 15 ಜನ ಸಿಬ್ಬಂದಿಯನ್ನು ಇಬ್ಬರು ನೌಕರರನ್ನು ಸರ್ಕಾರಿ ಜಿಲ್ಲಾ ಮುದ್ರಣಾಲಯ, ಶಿವಮೊಗ್ಗಕ್ಕೆ, 13 ಜನರನ್ನು ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು, ಇಲ್ಲಿಗೆ ವರ್ಗಾಯಿಸಿ, ಸರ್ಕಾರಿ ಜಿಲ್ಲಾ ಮುದ್ರಣಾಲಯ, ಮಂಗಳೂರು ಇದನ್ನು ತಾತ್ಕಾಲಿಕವಾಗಿ ಮುಚ್ಚಲು ಸರ್ಕಾರದ ಸೂಕ್ತ ಆದೇಶ ಹೊರಡಿಸುವಂತೆ ಸಹ ಕೋರಿರುತ್ತಾರೆ. ನಿರ್ದೇಶಕರು, ಮುದ್ರಣ, ಲೇಖನ ಸಾಮಗ್ರಿ ಮತ್ತು ಪ್ರಕಟಣೆಗಳ ಇಲಾಖೆ, ಬೆಂಗಳೂರು, ಇವರ ಪ್ರಸ್ತಾವನೆಯನ್ನು ಸರ್ಕಾರವು ಕೂಲಂಕುಷವಾಗಿ ಪರಿಶೀಲಿಸಿ ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಇಡಿ 621 ಎಲ್‌ಬಿಪಿ 2008, ದಿನಾಂಕ: 8ನೇ ಜೂನ್ 2009**

6. ಪ್ರಸ್ತಾವನೆಯಲ್ಲಿ ವಿವರಿಸಲಾದ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರಿ ಜಿಲ್ಲಾ ಮುದ್ರಣಾಲಯ, ಮಂಗಳೂರು, ಈ ಮುದ್ರಣಾಲಯವನ್ನು ಇನ್ನೂ ಮುಂದುವರೆಸುವುದು ಸೂಕ್ತವಲ್ಲವೆಂದು ಸರ್ಕಾರವು ತೀರ್ಮಾನಿಸಿ, ಈ ಆದೇಶಕ್ಕೆ ಲಗತ್ತಿಸಲಾಗಿರುವ ಅನುಬಂಧದಂತೆ ಸರ್ಕಾರಿ ಜಿಲ್ಲಾ ಮುದ್ರಣಾಲಯ, ಮಂಗಳೂರು ಇದನ್ನು ಹುದ್ದೆಗಳ ಸಮೇತ ಸರ್ಕಾರಿ ಕೇಂದ್ರ ಮುದ್ರಣಾಲಯ, ಮೈಸೂರು ರಸ್ತೆ, ಬೆಂಗಳೂರು, ಇಲ್ಲಿಗೆ ತಾತ್ಕಾಲಿಕವಾಗಿ ಸ್ಥಳಾಂತರಿಸಲು ಈ ಕೆಳಕಂಡ ಷರತ್ತುಗಳಿಗೆ ಒಳಪಟ್ಟು ಆದೇಶಿಸಲಾಗಿದೆ.

(ಅ) ಸ್ಥಳಾಂತರಕ್ಕೆ ಸಂಬಂಧಿಸಿದ ವೆಚ್ಚವನ್ನು ಇಲಾಖೆಗೆ 2009–10ನೇ ಸಾಲಿನಲ್ಲಿ ನಿಗದಿಪಡಿಸಿರುವ ಅನುದಾನದಲ್ಲಿಯೇ ಭರಿಸತಕ್ಕದ್ದು, ಯಾವುದೇ ಕಾರಣಕ್ಕೂ ಸರ್ಕಾರದಿಂದ ಹೆಚ್ಚುವರಿ ಅನುದಾನ ಕೋರುವಂತಿಲ್ಲ.

(ಆ) ಸ್ಥಳಾಂತರದ ಸಮಯದಲ್ಲಿ ಸರ್ಕಾರಿ ಆಸ್ತಿ ಹಾಗೂ ದಾಖಲೆಗಳಿಗೆ ಯಾವುದೇ ಹಾನಿಯಾಗದಂತೆ ಸೂಕ್ತ ಕ್ರಮ ಕೈಗೊಳ್ಳುವುದು.

(ಇ) ಸ್ಥಳಾಂತರಕ್ಕೆ ಸಂಬಂಧಿಸಿದಂತೆ ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ನಿಯಮಗಳನ್ನು ಕಟ್ಟುನಿಟ್ಟಾಗಿ ಪಾಲಿಸತಕ್ಕದ್ದು.

7. ಮುಂದುವರೆದಂತೆ ಸರ್ಕಾರಿ ಜಿಲ್ಲಾ ಮುದ್ರಣಾಲಯ, ಮಂಗಳೂರು, ಇಲ್ಲಿ ಕಾರ್ಯನಿರ್ವಹಿಸುತ್ತಿರುವ ಶ್ರೀ ಹರೀಶ್, ಅಗ್ರಕಾರ್ಮಿಕರು ಇವರನ್ನು ಸರ್ಕಾರಿ ಜಿಲ್ಲಾ ಮುದ್ರಣಾಲಯ, ಶಿವಮೊಗ್ಗ, ಇಲ್ಲಿ ಖಾಲಿ ಇರುವ ಹುದ್ದೆಗೆ ಸ್ಥಳ ನಿಯುಕ್ತಿಗೊಳಿಸಲಾಗಿದೆ ಹಾಗೂ ಸರ್ಕಾರಿ ಜಿಲ್ಲಾ ಮುದ್ರಣಾಲಯ, ಮಂಗಳೂರು, ಇಲ್ಲಿ ಕಾರ್ಯನಿರ್ವಹಿಸುತ್ತಿರುವ ಶ್ರೀ ಹರಿಕಟ್ಟೆ, ಪ್ರಥಮ ದರ್ಜೆ ಸಹಾಯಕರು, ಇವರನ್ನು ಹುದ್ದೆ ಸಮೇತ ಸರ್ಕಾರಿ ಜಿಲ್ಲಾ ಮುದ್ರಣಾಲಯ, ಶಿವಮೊಗ್ಗ, ಇಲ್ಲಿಗೆ ಸ್ಥಳಾಂತರಿಸಿ ಆದೇಶಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎಂ.ಎನ್. ಸೋಮಶೇಖರ್**

ಸರ್ಕಾರದ ಅಧೀನ ಕಾರ್ಯದರ್ಶಿ, ಶಿಕ್ಷಣ ಇಲಾಖೆ

**ಅನುಬಂಧ**

**(ಸರ್ಕಾರದ ಆದೇಶ ಸಂಖ್ಯೆ: ಇಡಿ 621 ಎಲ್‌ಬಿಪಿ 2008, ದಿನಾಂಕ: 08–06–2009)**

| ಕ್ರ. ಸಂ. | ಹುದ್ದೆಯ ವಿವರ | ಮಂಜೂರಾದ ಹುದ್ದೆಗಳ ಸಂಖ್ಯೆ | ಹಾಲಿ ಕೆಲಸ ನಿರ್ವಹಿಸುತ್ತಿರುವ ಅಧಿಕಾರಿ / ನೌಕರರ ಹೆಸರು ಶ್ರೀ / ಶ್ರೀಮತಿ | ಸ್ಥಳಾಂತರಿಸಲಾಗುತ್ತಿರುವ ಕಛೇರಿ |
|---|---|---|---|---|
| 1) | ಸಹಾಯಕ ನಿರ್ದೇಶಕರು (ತಾಂತ್ರಿಕ) | 1 | ಹೆಚ್.ಆರ್. ಪ್ರಕಾಶ್‌ನಾಯ್ಕ | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 2) | ಅಧೀಕ್ಷಕರು (ಲಿಪಿಕ) | 1 | ವಿ. ಶ್ರೀನಿವಾಸ | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 3) | ಪ್ರಥಮ ದರ್ಜೆ ಸಹಾಯಕರು (ಲಿಪಿಕ) | 1 | ಹರಿಕಟ್ಟೆ | ಸರ್ಕಾರಿ ಜಿಲ್ಲಾ ಮುದ್ರಣಾಲಯ, ಶಿವಮೊಗ್ಗ |

| ಕ್ರ. ಸಂ. | ಹುದ್ದೆಯ ವಿವರ | ಮಂಜೂರಾದ ಹುದ್ದೆಗಳ ಸಂಖ್ಯೆ | ಹಾಲಿ ಕೆಲಸ ನಿರ್ವಹಿಸುತ್ತಿರುವ ಅಧಿಕಾರಿ / ನೌಕರರ ಹೆಸರು ಶ್ರೀ / ಶ್ರೀಮತಿ | ಸ್ಥಳಾಂತರಿಸಲಾಗುತ್ತಿರುವ ಕಛೇರಿ |
|---|---|---|---|---|
| 4) | ದ್ವಿತೀಯ ದರ್ಜೆ ಸಹಾಯಕರು (ಲಿಪಿಕ) | 2 | ಇಲ್ಲ | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 5) | ಪ್ಯಾಕರ್ (ಲಿಪಿಕ) | 2 | 1) ಹೆಚ್.ಟಿ. ಗೋವಿಂದಯ್ಯ<br>2) ಜಿ.ಆರ್. ಜಯವರ್ಧನ | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 6) | ಮೇಲ್ವಿಚಾರಕರು | 1 | ಎನ್. ದಾಮೋದರ ಬಾಬು | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 7) | ಅಗ್ರಕಾರ್ಮಿಕರು | 1 | ಎಸ್. ಹರೀಶ್ | ಸರ್ಕಾರಿ ಜಿಲ್ಲಾ ಮುದ್ರಣಾಲಯ, ಶಿವಮೊಗ್ಗ |
| 8) | ಪ್ರಥಮ ದರ್ಜೆ ಸಹಾಯಕರು (ಕೈಗಾರಿಕೆ) | 1 | ಇಲ್ಲ | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 9) | ಹಿರಿಯ ಕರಡು ಪರೀಕ್ಷಕರು | 2 | ಇಲ್ಲ | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 10) | ದ್ವಿತೀಯ ದರ್ಜೆ ಸಹಾಯಕರು (ಕೈಗಾರಿಕೆ) | 3 | ಇಲ್ಲ | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 11) | ಹಿರಿಯ ಆಫ್‌ಸೆಟ್ ಮುದ್ರಕರು | 2 | 1) ಆರ್.ಕೆ. ದಶರಥ ಬಾಬು<br>2) ---- | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 12) | ಆಫ್‌ಸೆಟ್ ಮುದ್ರಕರು | 2 | 1) ಡಿ.ಹೆಚ್. ಪ್ರಭುಲಿಂಗ ಮಧುರೆ<br>2) --- | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 13) | ಸಹಾಯಕ ಆಫ್‌ಸೆಟ್ ಮುದ್ರಕರು | 10 | 1) ಆರ್.ಮಂಜುನಾಥ<br>9 ಹುದ್ದೆಗಳು ಖಾಲಿ ಇದೆ | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 14) | ಹಿರಿಯ ಅಕ್ಷರ ಸಂಯೋಜಕರು | 2 | 1) ಕೆ.ಆರ್. ಶಿವಾನಂದ<br>2) --- | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 15) | ಹಿರಿಯ ಬೈಂಡರ್ | 1 | ಯು. ಸುಬ್ರಾಯ | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 16) | ಹಿರಿಯ ಯಂತ್ರಚಾಲಕ | 1 | ಇಲ್ಲ | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 17) | ಸಹಾಯಕ ಡಿಟಿಪಿ ಆಪರೇಟರ್ | 2 | ಇಲ್ಲ | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 18) | ಸಹಾಯಕ ಬೈಂಡರ್ | 9 | 1) ಆರ್.ವೆಂಕಟೇಶ್<br>8 ಹುದ್ದೆಗಳು ಖಾಲಿ ಇದೆ | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 19) | ಪ್ಯಾಕರ್ (ಕೈಗಾರಿಕೆ) | 2 | ಇಲ್ಲ | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 20) | ಯಂತ್ರಚಾಲಕ | 2 | ಇಲ್ಲ | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 21) | ಸ್ವೀಪರ್ | 1 | ಇಲ್ಲ | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |
| 22) | ಕಂಪೋಸಿಟರ್ | 2 | 1) ಟಿ. ಸುರೇಶ್<br>2) ಎಂ. ಕರಿಯಪ್ಪ | ಸರ್ಕಾರಿ ಕೇಂದ್ರ ಮುದ್ರಣಾಲಯ, ಬೆಂಗಳೂರು |

**ಎಂ.ಎನ್. ಸೋಮಶೇಖರ್**

ಪಿ.ರ್. 1487 ಸರ್ಕಾರದ ಅಧೀನ ಕಾರ್ಯದರ್ಶಿ, ಶಿಕ್ಷಣ ಇಲಾಖೆ

**ತಿದ್ದುಪಡಿ ಆದೇಶ**

**ಸಂಖ್ಯೆ: ಇಡಿ 193 ಯೋಯೋಕ 2008, ಬೆಂಗಳೂರು, ದಿನಾಂಕ: 18ನೇ ಜೂನ್ 2009**

**ವಿಷಯ:** ಶಿಕ್ಷಣ ಇಲಾಖೆಯ ಉನ್ನತ ಶಿಕ್ಷಣ ವಲಯದಡಿ ಬರುವ ಕಾಲೇಜು ಶಿಕ್ಷಣ ಇಲಾಖೆಯಡಿ ಹೊಸ ಸರ್ಕಾರಿ ಪ್ರಥಮ ದರ್ಜೆ ಕಾಲೇಜುಗಳನ್ನು ಪ್ರಾರಂಭಿಸುವ ಬಗ್ಗೆ ಹೊರಡಿಸಿದ ಆದೇಶಕ್ಕೆ ತಿದ್ದುಪಡಿ ಮಾಡುವ ಬಗ್ಗೆ.

**ಉಲ್ಲೇಖ:** ಸರ್ಕಾರಿ ಆದೇಶ ಸಂಖ್ಯೆ ಇಡಿ 144 ಯೋಯೋಕ 2007, ದಿನಾಂಕ: 27.04.2007 [ಇಡಿ 66 ಸ್ಕೀಮರ (ಯುನಿಕ್) 2007, ದಿನಾಂಕ: 27.04.2007].

ಸರ್ಕಾರದ ಆದೇಶದ ಸಂಖ್ಯೆ: ಇಡಿ 144 ಯೋಯೋಕ 2007, ದಿನಾಂಕ: 27.04.2007ರ ಪುಟ: 09ರ ಕ್ರಮ ಸಂಖ್ಯೆ: 50ಕ್ಕೆ 2009–10ರ ಸಾಲಿನಿಂದ ಜಾರಿಗೆ ಬರುವಂತೆ ಈ ಕೆಳಕಂಡಂತೆ ತಿದ್ದುಪಡಿ ಮಾಡಿ ಆದೇಶಿಸಿದೆ.

| ಜಿಲ್ಲೆ | ಕ್ರಮ ಸಂಖ್ಯೆ | ಗ್ರಾಮದ ಹೆಸರು | ತಾಲ್ಲೂಕಿನ ಹೆಸರು |
|---|---|---|---|
| ಹಾವೇರಿ | 50 | ಬ್ಯಾಡಗಿ | ಬ್ಯಾಡಗಿ |

**ಎಂಬುದಕ್ಕೆ ಬದಲಾಗಿ**

| ಜಿಲ್ಲೆ | ಗ್ರಾಮದ ಹೆಸರು | ತಾಲ್ಲೂಕಿನ ಹೆಸರು |
|---|---|---|
| ಹಾವೇರಿ | ಚಿಕ್ಕಬಾಸೂರು | ಬ್ಯಾಡಗಿ |

ಉಳಿದ ಅಂಶಗಳು ಯಥಾವತ್ತಾಗಿ ಮುಂದುವರೆಯುತ್ತದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1490 **ಎಸ್.ಎಂ. ನಂದಕುಮಾರ್**

ಸರ್ಕಾರದ ಅಧೀನ ಕಾರ್ಯದರ್ಶಿ, ಉನ್ನತ ಶಿಕ್ಷಣ ಇಲಾಖೆ (ಯೋಜನೆ)

**ವಿಷಯ:** ಎ.ಇಡಿ ಮತ್ತು ಎ.ಟಿಸಿ ಪರೀಕ್ಷೆಗಳನ್ನು ಕನ್ನಡ ವಿಶ್ವವಿದ್ಯಾನಿಲಯ, ಹಂಪಿರವರ ಮೂಲಕ ನಡೆಸುವ ಬಗ್ಗೆ ಸರ್ಕಾರದ ಆದೇಶ.

**ಓದಲಾಗಿದೆ:** ಚೇತನ ಲಲಿತಕಲಾ ಮಹಾವಿದ್ಯಾಲಯ, ಗಿರಿನಗರ, ಬೆಂಗಳೂರು ಇಲ್ಲಿನ ಎಲ್ಲಾ ವಿದ್ಯಾರ್ಥಿಗಳು ದಿನಾಂಕ:30.05.2009ರ ಮನವಿ.

**ಪ್ರಸ್ತಾವನೆ:**

ಚೇತನ ಲಲಿತಕಲಾ ಮಹಾವಿದ್ಯಾಲಯ, ಗಿರಿನಗರ, ಬೆಂಗಳೂರು ಇವರು ಸರ್ಕಾರಕ್ಕೆ ಸಲ್ಲಿಸಿರುವ ಓದಲಾದ ದಿನಾಂಕ:30.05.2009ರ ಮನವಿ ಪತ್ರದಲ್ಲಿ 2008–09ನೇ ಸಾಲಿಗೆ ಒಟ್ಟು 60 ವಿದ್ಯಾರ್ಥಿಗಳು (ಇ.ಎಡಿ 50 + ಎ.ಟಿಸಿ 10) ಪ್ರವೇಶ ಪಡೆದಿದ್ದು, ದಿನಾಂಕ:22.12.2008 ರಂದು ಹೊರಡಿಸಿದ ನಿಯಮದಲ್ಲಿ ಕರ್ನಾಟಕ ಪ್ರೌಢಶಿಕ್ಷಣ ಮಂಡಳಿಯಿಂದ ಪರೀಕ್ಷೆಗಳಿಗೆ ಅವಕಾಶ ನೀಡಿರುವುದಾಗಿ ತಿಳಿದು ಬಂದಿದ್ದು, ಇಡೀ ಕರ್ನಾಟಕದಲ್ಲಿ ಎ.ಇಡಿ ಮತ್ತು ಎ.ಟಿಸಿ ಪರೀಕ್ಷೆಗಳು ಕನ್ನಡ ವಿಶ್ವವಿದ್ಯಾಲಯದ ಮೂಲಕವೇ ನಡೆಸುತ್ತಿದ್ದು, ಸದರಿ ವಿದ್ಯಾಲಯ ಮಾತ್ರ ಅದರ ವ್ಯಾಪ್ತಿಯಿಂದ ಹೊರಗುಳಿದಿರುವುದರಿಂದ 2009–10ನೇ ಶೈಕ್ಷಣಿಕ ಸಾಲಿನಿಂದ ಕನ್ನಡ ವಿಶ್ವವಿದ್ಯಾಲಯದ ಮೂಲಕವೇ ಎ.ಇಡಿ ಮತ್ತು ಎ.ಟಿಸಿ ಪರೀಕ್ಷೆಗಳನ್ನು ನಡೆಸುವಂತೆ ಸರ್ಕಾರದಲ್ಲಿ ಮನವಿ ಮಾಡಿರುತ್ತಾರೆ.

ಸದರಿ ಪ್ರಸ್ತಾವನೆಯನ್ನು ಸರ್ಕಾರವು ಪರಿಶೀಲಿಸಿ ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಇಡಿ 123 ಯೋಯೋಕ 2009, ಬೆಂಗಳೂರು, ದಿನಾಂಕ: 18ನೇ ಜೂನ್ 2009**

ಬೆಂಗಳೂರಿನ ಗಿರಿನಗರದಲ್ಲಿರುವ ಚೇತನ ಕಲಾ ಮಹಾವಿದ್ಯಾಲಯವು 2009–10ನೇ ಶೈಕ್ಷಣಿಕ ಸಾಲಿನಿಂದ ಎ.ಇಡಿ ಮತ್ತು ಎ.ಟಿಸಿ ಪರೀಕ್ಷೆಗಳನ್ನು ಹಂಪಿ ಕನ್ನಡ ವಿಶ್ವವಿದ್ಯಾಲಯದ ಮೂಲಕ ನಡೆಸಲು ಸರ್ಕಾರದ ಅನುಮತಿ ನೀಡಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1491 **ಎಸ್.ಎಂ. ನಂದಕುಮಾರ್**

ಸರ್ಕಾರದ ಅಧೀನ ಕಾರ್ಯದರ್ಶಿ, ಉನ್ನತ ಶಿಕ್ಷಣ ಇಲಾಖೆ (ಯೋಜನೆ)

**ವಿಷಯ:** ಹಾಸನದಲ್ಲಿ ಹೊಸದಾಗಿ ಪ್ರಾರಂಭವಾಗಿರುವ ಸರ್ಕಾರಿ ಪದವಿ ಪೂರ್ವ ಕಾಲೇಜು ವಿದ್ಯಾನಗರದ ಕಟ್ಟಡ ಬಾಡಿಗೆ ನೀಡುವ ಬಗ್ಗೆ.

**ಓದಲಾಗಿದೆ:** ಆಯುಕ್ತರು, ಪದವಿ ಪೂರ್ವ ಶಿಕ್ಷಣ ಇಲಾಖೆ, ಬೆಂಗಳೂರುರವರ ಪತ್ರ ಸಂಖ್ಯೆ: ಪಪೂಶಿಇ/ಕಟ್ಟಡ/ಬಾಡಿಗೆ–01/07–08/ದಿನಾಂಕ:26.05.2009.

**ಪ್ರಸ್ತಾವನೆ:**

1. ಮೇಲೆ ಓದಲಾದ ಪತ್ರದಲ್ಲಿ ಆಯುಕ್ತರು, ಪದವಿ ಪೂರ್ವ ಶಿಕ್ಷಣ ಇಲಾಖೆ, ಬೆಂಗಳೂರುರವರು ಹಾಸನ ಜಿಲ್ಲೆ, ಹಾಸನದಲ್ಲಿ 2007–08ನೇ ಸಾಲಿಗೆ ಹೊಸದಾಗಿ ಮಂಜೂರಾಗಿ ಪ್ರಾರಂಭವಾಗಿರುವ ಸರ್ಕಾರಿ ಪದವಿ ಪೂರ್ವ ಕಾಲೇಜು, ವಿದ್ಯಾನಗರ, ಬಾಲಕಿಯರ ಸ.ಪ.ಪೂ.ಕಾಲೇಜು, [ವಿಭಜಿತ] ಹಾಸನ ಇದಕ್ಕೆ ಸ್ವಂತ ಕಟ್ಟಡ ಇಲ್ಲದೇ

ಇರುವುದರಿಂದ ಖಾಸಗಿ ಕಟ್ಟಡವನ್ನು ಬಾಡಿಗೆ ಆಧಾರದ ಮೇಲೆ ಪಡೆದಿದ್ದು, ಅದಕ್ಕೆ ಬಾಡಿಗೆ ನೀಡಲು ಸರ್ಕಾರವು ತನ್ನ ಆದೇಶ ಸಂಖ್ಯೆ ಇಡಿ 261 ಯೋಸಕ 2008, ದಿನಾಂಕ:06.03.2009ರಂದು ಆದೇಶ ನೀಡಲಾಗಿತ್ತು. ಆದರೆ ಬಿಡುಗಡೆ ಮಾಡಲಾದ ಲೆಕ್ಕ ಶೀರ್ಷಿಕೆಯಲ್ಲಿ ಅನುದಾನ ಲಭ್ಯವಿಲ್ಲದ ಕಾರಣ ಬಾಡಿಗೆ ಹಣವನ್ನು ಬಿಡುಗಡೆ ಮಾಡಲಾಗಲಿಲ್ಲವೆಂದು ತಿಳಿಸಿ ಈಗ 2009–10ನೇ ಸಾಲಿನ ಅನುದಾನದಲ್ಲಿ ಪಾವತಿಸಲು ಅನುಮತಿ ನೀಡುವಂತೆ ಕೋರಿರುತ್ತಾರೆ. ಅಲ್ಲದೇ ಸರ್ಕಾರಿ ಪದವಿ ಪೂರ್ವ ಕಾಲೇಜು ಹಾಸನ ಈ ಕಾಲೇಜಿಗೆ ದಿನಾಂಕ: 23.07.07 ರಿಂದ 31.03.2009ರವರೆಗೆ ಉಳಿಕೆ ಬಾಡಿಗೆ ಬಾಕಿ ಒಟ್ಟು 6.09ಲಕ್ಷರೂಗಳನ್ನು ಬಿಡುಗಡೆ ಮಾಡುವಂತೆ ಕೋರಿರುತ್ತಾರೆ.

2. ಸದರಿ ಪ್ರಸ್ತಾವನೆಯನ್ನು ಪರಿಶೀಲಿಸಿದ ಸರ್ಕಾರವು ಈ ಕೆಳಕಂಡಂತೆ ಆದೇಶಿಸುತ್ತದೆ.

**ಸರ್ಕಾರಿ ಆದೇಶ ಸಂಖ್ಯೆ: ಇಡಿ: 261: ಯೋಸಕ 2008 ಬೆಂಗಳೂರು, ದಿನಾಂಕ: 17ನೇ ಜೂನ್ 2009**

**[ನಿಡಿ: 80 : ಸ್ವೀಮರ(ಯುನಿಕ್) 2009, ದಿನಾಂಕ: 17–06–2009]**

3. 2007–08ನೇ ಸಾಲಿಗೆ ಹಾಸನ ಜಿಲ್ಲೆ ಹಾಸನದ ವಿದ್ಯಾನಗರದಲ್ಲಿ ಹೊಸದಾಗಿ ಪ್ರಾರಂಬಿಸಲಾದ ಸರ್ಕಾರಿ ಪದವಿ ಪೂರ್ವ ಕಾಲೇಜಿನ ತರಗತಿಗಳನ್ನು ನಡೆಸಲು ಬಾಡಿಗೆ ಪಡೆದಿರುವ ಖಾಸಗಿ ಕಟ್ಟಡವಾದ ಮಂಗಳಾ ದೇವಿ ಭವನ, ಸಾಲಗಾಮೆ ರಸ್ತೆ, ಹಾಸನದ ಕಟ್ಟಡ ಬಾಡಿಗೆ ಬಾಕಿಯನ್ನು ದಿನಾಂಕ:23.07.07 ರಿಂದ 31.03.2009 ರ ತನಕ ಮಾಹೆಯಾನ 30000.,00 ರೂಗಳಂತೆ [ಮೂವತ್ತು ಸಾವಿರ ರೂಪಾಯಿಗಳು ಮಾತ್ರ] ಒಟ್ಟು 6,09,000ರೂಗಳನ್ನು [ಆರು ಲಕ್ಷ ಒಂಭತ್ತು ಸಾವಿರ ರೂಪಾಯಿಗಳು ಮಾತ್ರ] ಭರಿಸಲು ನಿರ್ದೇಶಕರು, ಪದವಿ ಪೂರ್ವ ಶಿಕ್ಷಣ ಇಲಾಖೆ, ಬೆಂಗಳೂರು ಇವರಿಗೆ ಸರ್ಕಾರವು ಅನುಮತಿ ನೀಡಿದೆ.

4. ಸದರಿ ಮೊತ್ತವನ್ನು 2009–10ನೇ ಸಾಲಿಗೆ ಲೆಕ್ಕಶೀರ್ಷಿಕೆ 2202–02–109–0–13–071[ಯೋಜನೇತರದಡಿ] ಒದಗಿಸಲಾಗಿರುವ ಅನುದಾನದ ಮಿತಿಯೊಳಗೇ ಭರಿಸತಕ್ಕದ್ದು.

5. ಸದರಿ ಆದೇಶವನ್ನು ಶಿಕ್ಷಣ ಇಲಾಖೆಯ ಆಂತರಿಕ ಆರ್ಥಿಕ ಇಲಾಖೆಯ ಅನಧಿಕೃತ ಟಿಪ್ಪಣಿ ಸಂಖ್ಯೆ ಶಿ.ಇ: 1195: ಐ.ಎಫ್(ಬಿಎ) 2009/ದಿನಾಂಕ:01.06.2009 ರಲ್ಲಿ ನೀಡಿರುವ ಸಹಮತಿಯನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಐ.ಎಫ್. ಮಾಗಿ**

ಪಿ.ಆರ್. 1493

ವಿಶೇಷಾಧಿಕಾರಿಗಳು ಹಾಗೂ ಪದನಿಮಿತ್ತ

ಸರ್ಕಾರದ ಅಧೀನ ಕಾರ್ಯದರ್ಶಿ, ಶಿಕ್ಷಣ ಇಲಾಖೆ (ಯೋಜನೆ)

**ವಿಷಯ:** ಲೋಕಶಿಕ್ಷಣ ನಿರ್ದೇಶನಾಲಯ ಮತ್ತು ರಾಜ್ಯ ಸಾಕ್ಷರತಾ ಮಿಷನ್ ಪ್ರಾಧಿಕಾರದ ಇ–ಆಡಳಿತ ವಿಭಾಗ ಮತ್ತು ಕಚೇರಿಯ ಉಪಯೋಗಕ್ಕಾಗಿ ಗಣಕ ಮತ್ತಿತರ ಯಂತ್ರಗಳನ್ನು ಖರೀದಿಸಲು ಅನುಮತಿ ನೀಡುವ ಬಗ್ಗೆ.

**ಓದಲಾಗಿದೆ:** 1) ನಿರ್ದೇಶಕರು, ಲೋಕಶಿಕ್ಷಣ ಇಲಾಖೆ, ಬೆಂಗಳೂರು ರವರ ಪತ್ರ ಸಂ: ಸಿ 11:ಕೆಎಸ್ಎಲ್ ಎಂಎಸಿಆರ್: 45:2008–09/ದಿನಾಂಕ:25.4.2009.

2) ಕಾರ್ಯದರ್ಶಿಗಳು (ಇ–ಆಡಳಿತ), ಡಿಪಿಎಆರ್ (ಎಆರ್) ರವರ ಸುತ್ತೋಲೆ ಸಂಖ್ಯೆ:ಡಿಪಿಎಆರ್ 39 ಇಜಿವಿ 2004, ದಿನಾಂಕ:13.6.2005.

**ಪ್ರಸ್ತಾವನೆ:**

ಮೇಲೆ ಓದಲಾದ ಪತ್ರದಲ್ಲಿ ನಿರ್ದೇಶಕರು, ಲೋಕಶಿಕ್ಷಣ ನಿರ್ದೇಶನಾಲಯ, ಬೆಂಗಳೂರುರವರು, ಲೋಕ ಶಿಕ್ಷಣ ನಿರ್ದೇಶನಾಲಯ ಮತ್ತು ರಾಜ್ಯ ಸಾಕ್ಷರತಾ ಮಿಷನ್, ಪ್ರಾಧಿಕಾರದ ಇ–ಆಡಳಿತ ವಿಭಾಗ ಮತ್ತು ಕಚೇರಿಯ ಉಪಯೋಗಕ್ಕಾಗಿ 03 ಗಣಕ ಯಂತ್ರಗಳು, 2 ಲ್ಯಾಪ್ ಟಾಪ್‌ಗಳು, 3 ಲೇಸರ್ ಪ್ರಿಂಟರ್ಸ್‌ಗಳು ಹಾಗೂ ಒಂದು ಝುರಾಕ್ಸ್ ಯಂತ್ರಗಳು ಅಗತ್ಯವಾಗಿ ಬೇಕಾಗಿರುವುದರಿಂದ ಇವುಗಳನ್ನು ಡಿ.ಜಿ.ಎಸ್ ಮತ್ತು ಡಿ ದರಗಳನ್ನು ಹೊಂದಿರುವ ಸಂಸ್ಥೆಗಳಿಂದ ಒಟ್ಟಾರೆ 4.20057/– ಲಕ್ಷ ರೂ.ಗಳಲ್ಲಿ ಖರೀದಿಸಲು ಸರ್ಕಾರದ ಅನುಮತಿಯನ್ನು ಕೋರಿರುತ್ತಾರೆ. ಇದಕ್ಕೆ ತಗಲುವ ವೆಚ್ಚವನ್ನು ರಾಜ್ಯ ಸಾಕ್ಷರತಾ ಮಿಷನ್ ಪ್ರಾಧಿಕಾರದಲ್ಲಿರುವ ಶೇ.2 ರ ಆಡಳಿತಾತ್ಮಕ ವೆಚ್ಚದಲ್ಲಿ ಭರಿಸುವುದಾಗಿ ತಿಳಿಸಿರುತ್ತಾರೆ.

ಮೇಲೆ (2) ರಲ್ಲಿ ಓದಲಾದ ಸರ್ಕಾರದ ಸುತ್ತೋಲೆಯಲ್ಲಿ ಇ–ಆಡಳಿತಕ್ಕೆ ಬೇಕಾಗುವ ಗಣಕ ಯಂತ್ರ ಮುಂತಾದ ಯಂತ್ರಗಳನ್ನು ಖರೀದಿಸುವ ಬಗ್ಗೆ ಮಾರ್ಗಸೂಚಿಗಳನ್ನು ನೀಡಲಾಗಿದೆ.

ಸದರಿ ಪ್ರಸ್ತಾವನೆಯನ್ನು ಸರ್ಕಾರದಲ್ಲಿ ಪರಿಶೀಲಿಸಿ ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಇಡಿ: 91 ಯೋಯೋಕ 2009, ಬೆಂಗಳೂರು, ದಿನಾಂಕ: 30ನೇ ಜೂನ್ 2009**
**[ಇಡಿ: 84 ಸ್ವೀಮರ(ಯುನಿಕ್) 2009, ದಿನಾಂಕ: 30.06.2009]**

2009–10ನೇ ಸಾಲಿಗೆ ಲೋಕ ಶಿಕ್ಷಣ ನಿರ್ದೇಶನಾಲಯ ಮತ್ತು ರಾಜ್ಯ ಸಾಕ್ಷರತಾ ಮಿಷನ್ ಪ್ರಾಧಿಕಾರದ ಇ–ಆಡಳಿತ ವಿಭಾಗ ಮತ್ತು ಕಚೇರಿಯ ಉಪಯೋಗಕ್ಕಾಗಿ 03 ಗಣಕ ಯಂತ್ರಗಳು, 02 ಲ್ಯಾಪ್‌ಟಾಪ್‌ಗಳು, 03 ಲೇಸರ್ ಪ್ರಿಂಟರ್ಸ್‌ಗಳು ಹಾಗೂ ಒಂದು ಝೆರಾಕ್ಸ್ ಯಂತ್ರವನ್ನು 4.20557 ಲಕ್ಷ ರೂಪಾಯಿಗಳ (ನಾಲ್ಕು ಲಕ್ಷ ಇಪ್ಪತ್ತು ಸಾವಿರದ ಐದುನೂರಾ ಐವತ್ತೇಳು ರೂಪಾಯಿಗಳು ಮಾತ್ರ) ಮಿತಿಯೊಳಗೆ ಡಿ.ಜಿ.ಎಸ್ ಮತ್ತು ಡಿ ದರಗಳನ್ನು ಹೊಂದಿರುವ ಸಂಸ್ಥೆಗಳಿಂದ ಅಥವಾ ಕರ್ನಾಟಕ ಪಾರದರ್ಶಕ ಕಾಯ್ದೆಯಡಿಯ ನಿಯಮಗಳನ್ನು ಪಾಲಿಸಿ ಖರೀದಿಸಲು ಈ ಕೆಳಕಂಡ ಷರತ್ತನ್ನು ವಿಧಿಸಿ ನಿರ್ದೇಶಕರು, ಲೋಕ ಶಿಕ್ಷಣ ನಿರ್ದೇಶನಾಲಯ, ಬೆಂಗಳೂರುರವರಿಗೆ ಅನುಮತಿ ನೀಡಿದೆ.

**ಷರತ್ತುಗಳು:–**

ಅ. ಸದರಿ ಪ್ರಸ್ತಾವನೆಯು ಇಲಾಖೆಯ ಅಂಗೀಕೃತ ಇ–ಆಡಳಿತ ಕಾರ್ಯಯೋಜನೆಯಲ್ಲಿ ಅನುಮೋದಿತವಾಗಿರಬೇಕು.

ಆ. ಕಾನ್‌ಫಿಗರೇಷನ್ ಬಗ್ಗೆ ಇ–ಆಡಳಿತ ಇಲಾಖೆಯು ಅಂಗೀಕರಿಸುವ ಕಾನ್‌ಫಿಗರೇಷನ್‌ನ್ನು ಪಡೆದು ಕ್ರಮ ವಹಿಸಬೇಕು.

ಮೇಲ್ಕಂಡ ಮೊತ್ತವನ್ನು ರಾಜ್ಯ ಸಾಕ್ಷರತಾ ಮಿಷನ್ ಪ್ರಾಧಿಕಾರದಲ್ಲಿರುವ ಶೇ.2 ರ ಆಡಳಿತಾತ್ಮಕ ವೆಚ್ಚದಲ್ಲಿ ನಿಯಮಾನುಸಾರ ಬಳಸಲು ಸೂಚಿಸಿದೆ.

ಸದರಿ ಆದೇಶವನ್ನು ಶಿಕ್ಷಣ ಇಲಾಖೆಯ ಆಂತರಿಕ ಆರ್ಥಿಕ ಇಲಾಖೆಯ ಅನಧಿಕೃತ ಟಿಪ್ಪಣಿ ಸಂಖ್ಯೆ: ಶಿ.ಇ:1152ಐಎಫ್(ಬಿಎ) 2009/ದಿನಾಂಕ:27.5.2009 ರಲ್ಲಿನ ಸಹಮತಿಯನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಐ.ಎಫ್. ಮಾಗಿ**

ಪಿ.ಆರ್. 1494

ವಿಶೇಷಾಧಿಕಾರಿಗಳು ಹಾಗೂ ಪದನಿಮಿತ್ತ
ಸರ್ಕಾರದ ಅಧೀನ ಕಾರ್ಯದರ್ಶಿ, ಶಿಕ್ಷಣ ಇಲಾಖೆ (ಯೋಜನೆ)

**ವಿಷಯ:** 2009–10ನೇ ಸಾಲಿಗೆ ಶಿಕ್ಷಣ ಇಲಾಖೆಯಲ್ಲಿ ಸೇವೆ ಸಲ್ಲಿಸುತ್ತಿರುವ ಅಧಿಕಾರಿ/ಸಿಬ್ಬಂದಿ ವರ್ಗದವರಿಗೆ ವೈದ್ಯಕೀಯ ವೆಚ್ಚವನ್ನು ಮರು ಪಾವತಿಸುವ ಬಗ್ಗೆ.

**ಓದಲಾಗಿದೆ:** 1) ಆರ್ಥಿಕ ಇಲಾಖೆಯ ಸುತ್ತೋಲೆ ಸಂಖ್ಯೆ ಆಇ 07 ಬಿ.ಪಿ.ಇ 2009, ದಿನಾಂಕ: 30.04.2009.

2) ಶಿಕ್ಷಣ ಇಲಾಖೆಯ ಆಂತರಿಕ ಆರ್ಥಿಕ ಸಲಹೆಗಾರರ ಅ.ಟಿ.ಸಂಖ್ಯೆ ಶಿಇ 1102 ಐಎಫ್ (ಬಿ & ಎ) 2009, ದಿನಾಂಕ:30.05.2009.

3) ನಿರ್ದೇಶಕರು, ರಾಜ್ಯ ಶೈಕ್ಷಣಿಕ ಸಂಶೋಧನೆ ಮತ್ತು ತರಬೇತಿ ಇಲಾಖೆರವರ ಪತ್ರ ಸಂಖ್ಯೆ ಒಬ4/ವೈ.ವೆ.ಮ.ಪಾ/2009–10/ದಿನಾಂಕ: 20.05.2009.

4) ಆಯುಕ್ತರು, ಸಾರ್ವಜನಿಕ ಶಿಕ್ಷಣ ಇಲಾಖೆ, ಬೆಂಗಳೂರು ರವರ ಪತ್ರ ಸಂಖ್ಯೆ ಆಯವ್ಯಯ 1 ವೈ ಮ ಪಾ ವೆಚ್ಚ ಆ ಬಿಡುಗಡೆ 10/ 2009–10, ದಿನಾಂಕ: 24.06.2009.

5) ನಿರ್ದೇಶಕರು, ಲೋಕ ಶಿಕ್ಷಣ ಇಲಾಖೆ ರವರ ಪತ್ರ ಸಂಖ್ಯೆ ಎ4:ಡಿಎಂಇ:ವೈ.ವೆ.ಮ.ಪಾ–10/ 09–10/ದಿನಾಂಕ:02.06.2009.

**ಪ್ರಸ್ತಾವನೆ:**

(1) ಮೇಲೆ (1) ರಲ್ಲಿ ಓದಲಾದ ಆರ್ಥಿಕ ಇಲಾಖೆಯ ಸುತ್ತೋಲೆಯಲ್ಲಿ 2009–10ನೇ ಸಾಲಿಗೆ ರಾಜ್ಯ ವಲಯದಡಿ ಲೆಕ್ಕಶೀರ್ಷಿಕೆ:–2202–80–800–0–38–021ರಲ್ಲಿ ಯೋಜನೆಯಡಿ 9.00ಲಕ್ಷ ರೂಪಾಯಿಗಳು ಹಾಗೂ ಯೋಜನೇತರದಡಿ 26.00 ಲಕ್ಷರೂಗಳನ್ನು ಒದಗಿಸಿರುತ್ತಾರೆ.

(2) ಮೇಲೆ (1) ರಲ್ಲಿ ಓದಲಾದ ಶಿಕ್ಷಣ ಇಲಾಖೆಯ ಆಂತರಿಕ ಆರ್ಥಿಕ ಸಲಹೆಗಾರರ ಪತ್ರದಲ್ಲಿ 2009–10ನೇ ಸಾಲಿಗೆ ರಾಜ್ಯ ವಲಯದಡಿ ಲೆಕ್ಕಶೀರ್ಷಿಕೆ:–2202–80–800–0–38–021ರಲ್ಲಿ ಯೋಜನೆಯಡಿ 9.00 ಲಕ್ಷ ರೂಪಾಯಿಗಳು ಹಾಗೂ ಯೋಜನೇತರದಡಿ 26.00 ಲಕ್ಷ ರೂ.ಗಳನ್ನು ಆರ್ಥಿಕ ಇಲಾಖೆಯು ಒದಗಿಸಿದ್ದು, ಅದನ್ನು ಎಲ್ಲ ಇಲಾಖಾ ಮುಖ್ಯಸ್ಥರುಗಳಿಂದ ಬೇಡಿಕೆ ಪಡೆದು ನಿಗದಿಪಡಿಸಿರುವ ಅನುದಾನವನ್ನು ಮರುಹಂಚಿಕೆ ಮಾಡಲು ಕ್ರಮ ಕೈಗೊಳ್ಳುವಂತೆ ಸೂಚಿಸಿರುತ್ತಾರೆ.

(3) ಮೇಲೆ (3) ರ ಪತ್ರದಲ್ಲಿ ನಿರ್ದೇಶಕರು, ರಾಜ್ಯ ಶೈಕ್ಷಣಿಕ ಸಂಶೋಧನೆ ಮತ್ತು ತರಬೇತಿ ಇಲಾಖೆ ಬೆಂಗಳೂರುರವರು ಅವರ ಕಛೇರಿಯಲ್ಲಿ ಸೇವೆ ಸಲ್ಲಿಸುತ್ತಿರುವ ಅಧಿಕಾರಿಗಳು/ಸಿಬ್ಬಂದಿ ವರ್ಗದವರಿಗೆ ವೈದ್ಯಕೀಯ

ವೆಚ್ಚದ ಹಣವನ್ನು ಮರುಪಾವತಿಗಾಗಿ, 2009–10ನೇ ಸಾಲಿಗೆ ರಾಜ್ಯ ವಲಯದಡಿ ಲೆಕ್ಕಶೀರ್ಷಿಕೆ:–2202–80–800–0–38–021ರಲ್ಲಿ ಯೋಜನೆಯಡಿ 9.00 ಲಕ್ಷರೂಪಾಯಿಗಳು ಹಾಗೂ ಯೋಜನೇತರದಡಿ 26.00 ಲಕ್ಷರೂಗಳನ್ನು ಒದಗಿಸಿದ್ದು, ಅದರಲ್ಲಿ 6.00 ಲಕ್ಷರೂಪಾಯಿಗಳನ್ನು ಬಿಡುಗಡೆ ಮಾಡುವಂತೆ ಕೋರಿರುತ್ತಾರೆ. ಎಲ್ಲಾ ಹುದ್ದೆಗಳು ಯೋಜನೇತರದಡಿ ಇರುತ್ತದೆ ಎಂದು ತಿಳಿಸಿರುತ್ತಾರೆ.

(4) ಮೇಲೆ (4)ರಲ್ಲಿ ಓದಲಾದ ಪತ್ರದಲ್ಲಿ ಆಯುಕ್ತರು, ಸಾರ್ವಜನಿಕ ಶಿಕ್ಷಣ ಇಲಾಖೆ, ಬೆಂಗಳೂರುರವರು, ಅವರ ಕಛೇರಿಯಲ್ಲಿ ಸೇವೆ ಸಲ್ಲಿಸುತ್ತಿರುವ ಅಧಿಕಾರಿಗಳು/ ಸಿಬ್ಬಂದಿ ವರ್ಗದವರಿಗೆ ವೈದ್ಯಕೀಯ ವೆಚ್ಚದ ಹಣವನ್ನು ಮರುಪಾವತಿಗಾಗಿ, 2009–10ನೇ ಸಾಲಿಗೆ ರಾಜ್ಯ ವಲಯದಡಿ ಲೆಕ್ಕಶೀರ್ಷಿಕೆ:–2202–80–800–0–38–021ರಲ್ಲಿ ಯೋಜನೆಯಡಿ 9.00 ಲಕ್ಷರೂಪಾಯಿಗಳು ಹಾಗೂ ಯೋಜನೇತರದಡಿ 26.00 ಲಕ್ಷರೂಗಳನ್ನು ಒದಗಿಸಿದ್ದು, ಅದರಲ್ಲಿ 34.00 ಲಕ್ಷರೂಪಾಯಿಗಳನ್ನು ಈ ಕೆಳಕಂಡ ಇಲಾಖೆಗಳಿಗೆ ಹಂಚಿಕೆ ಮಾಡಿ ಬಿಡುಗಡೆ ಮಾಡುವಂತೆ ಕೋರಿರುತ್ತಾರೆ. ಎಲ್ಲಾ ಹುದ್ದೆಗಳು ಯೋಜನೇತರದಲ್ಲಿದೆ ಎಂದು ವರದಿ ಮಾಡಿರುತ್ತಾರೆ.

| ಕ್ರ. ಸಂ. | ಇಲಾಖೆಯ ಹೆಸರು | ಕೋರಿರುವ ಅನುದಾನ [ಲಕ್ಷ ರೂಗಳಲ್ಲಿ] |
|---|---|---|
| 1 | ಆಯುಕ್ತರ ಕಛೇರಿ, ಸಾರ್ವಜನಿಕ ಶಿಕ್ಷಣ ಇಲಾಖೆ, ಬೆಂಗಳೂರು | 20.00 |
| 2 | ನಿರ್ದೇಶಕರು, ಸಂಶೋಧನೆ ಮತ್ತು ತರಬೇತಿ ಇಲಾಖೆ | 6.00 |
| 3 | ನಿರ್ದೇಶಕರು, ಉರ್ದು ಮತ್ತು ಇತರೆ ಭಾಷಾ ಅಲ್ಪ ಸಂಖ್ಯಾತ ಶಾಲೆಗಳ ನಿರ್ದೇಶನಾಲಯ | 2.00 |
| 4 | ಶಾಲೆಗಳ ಮುಖ್ಯ ವೈದ್ಯಕೀಯ ಪರಿವೀಕ್ಷಕರು, ಆಯುಕ್ತರ ಕಛೇರಿ, ಸಾರ್ವಜನಿಕ ಶಿಕ್ಷಣ ಇಲಾಖೆ, ಬೆಂಗಳೂರು | 1.00 |
| 5 | ಪ್ರಾಂಶುಪಾಲರು, ಸರ್ಕಾರಿ ಚಾಮರಾಜೇಂದ್ರ ಸಂಸ್ಕೃತ ಕಾಲೇಜು, ಚಾಮರಾಜಪೇಟೆ | 5.00 |
| | **ಒಟ್ಟು** | **34.00** |

(5) ಮೇಲೆ (5) ರಲ್ಲಿ ಓದಲಾದ ಪತ್ರದಲ್ಲಿ ನಿರ್ದೇಶಕರು, ಲೋಕ ಶಿಕ್ಷಣ ಇಲಾಖೆ ಬೆಂಗಳೂರು ರವರು, ಅವರ ಕಛೇರಿಯಲ್ಲಿ ಸೇವೆ ಸಲ್ಲಿಸುತ್ತಿರುವ ಅಧಿಕಾರಿಗಳು/ಸಿಬ್ಬಂದಿ ವರ್ಗದವರಿಗೆ ವೈದ್ಯಕೀಯ ವೆಚ್ಚದ ಹಣವನ್ನು ಮರುಪಾವತಿಗಾಗಿ, 2009–10ನೇ ಸಾಲಿಗೆ ರಾಜ್ಯ ವಲಯದಡಿ ಲೆಕ್ಕಶೀರ್ಷಿಕೆ:–2202–80–800–0–38–021ರಲ್ಲಿ ಯೋಜನೆಯಡಿ 9.00 ಲಕ್ಷರೂಪಾಯಿಗಳು ಹಾಗೂ ಯೋಜನೇತರದಡಿ 26.00 ಲಕ್ಷರೂಗಳನ್ನು ಒದಗಿಸಿದ್ದು, ಅದರಲ್ಲಿ 1.50 ಲಕ್ಷರೂಗಳನ್ನು ಬಿಡುಗಡೆ ಮಾಡುವಂತೆ ಕೋರಿರುತ್ತಾರೆ.

(6) ಸದರಿ ಪ್ರಸ್ತಾವನೆಯನ್ನು ಪರಿಶೀಲಿಸಿದ ಸರ್ಕಾರವು ಈ ಕೆಳಕಂಡಂತೆ ಆದೇಶಿಸುತ್ತದೆ.

**ಸರ್ಕಾರಿ ಆದೇಶ ಸಂಖ್ಯೆ: ಇಡಿ: 117 : ಯೋಸಕ 2009, ಬೆಂಗಳೂರು, ದಿನಾಂಕ: 30ನೇ ಜೂನ್ 2009**

**[ಇಡಿ: 85 : ಸ್ವೀಮರ(ಯುನಿಕ್) 2009, ದಿನಾಂಕ: 30–06–2009]**

(7) 2009–10ನೇ ಸಾಲಿಗೆ ರಾಜ್ಯ ವಲಯದಡಿ ಲೆಕ್ಕಶೀರ್ಷಿಕೆ:–2202–80–800–0–38–021ರ ಯೋಜನೇತರ ದಡಿ ಒದಗಿಸಲಾದ 26.00 ಲಕ್ಷರೂಗಳಲ್ಲಿ 5.00 ಲಕ್ಷರೂಪಾಯಿಗಳನ್ನು [ಐದು ಲಕ್ಷ ರೂಪಾಯಿಗಳು ಮಾತ್ರ] ರಾಜ್ಯ ಶೈಕ್ಷಣಿಕ ಸಂಶೋಧನೆ ಮತ್ತು ತರಬೇತಿ ಇಲಾಖೆಯಲ್ಲಿ ಯೋಜನೇತರದಡಿ ಸೇವೆ ಸಲ್ಲಿಸುತ್ತಿರುವ ಅಧಿಕಾರಿಗಳು/ ಸಿಬ್ಬಂದಿ ವರ್ಗದವರಿಗೆ ವೈದ್ಯಕೀಯ ವೆಚ್ಚದ ಹಣ ಮರುಪಾವತಿ ಭರಿಸಲು ನಿರ್ದೇಶಕರು, ರಾಜ್ಯ ಶೈಕ್ಷಣಿಕ ಸಂಶೋಧನೆ ಮತ್ತು ತರಬೇತಿ ಇಲಾಖೆ, ಬೆಂಗಳೂರು ಇವರಿಗೆ ಅನುಮತಿ ನೀಡಿದೆ.

(8) ರಾಜ್ಯ ವಲಯದಡಿ ಲೆಕ್ಕಶೀರ್ಷಿಕೆ:–2202–80–800–0–38–021ರ ಯೋಜನೇತರದಡಿ ಒದಗಿಸಲಾದ 26.00 ಲಕ್ಷರೂಗಳಲ್ಲಿ 1.50 ಲಕ್ಷರೂಪಾಯಿಗಳನ್ನು [ಒಂದು ಲಕ್ಷದ ಐವತ್ತು ಸಾವಿರ ರೂಪಾಯಿಗಳು ಮಾತ್ರ] ಲೋಕ ಶಿಕ್ಷಣ ಇಲಾಖೆಯಲ್ಲಿ ಯೋಜನೇತರದಡಿ ಸೇವೆ ಸಲ್ಲಿಸುತ್ತಿರುವ ಅಧಿಕಾರಿಗಳು/ ಸಿಬ್ಬಂದಿ ವರ್ಗದವರಿಗೆ ವೈದ್ಯಕೀಯ ವೆಚ್ಚದ ಹಣ ಮರುಪಾವತಿ ಭರಿಸಲು ನಿರ್ದೇಶಕರು, ಲೋಕಶಿಕ್ಷಣ ನಿರ್ದೇಶನಾಲಯ ಬೆಂಗಳೂರು ಇವರಿಗೆ ಅನುಮತಿ ನೀಡಿದೆ.

(9) ರಾಜ್ಯ ವಲಯದಡಿ ಲೆಕ್ಕೀರ್ಷಿಕೆ:2202–80–800–0–38–021ರ ಯೋಜನೇತರದಡಿ ಒದಗಿಸಲಾದ 26.00 ಲಕ್ಷರೂಗಳಲ್ಲಿ, 10.00 ಲಕ್ಷರೂಗಳು [ಹತ್ತು ಲಕ್ಷರೂಪಾಯಿಗಳು ಮಾತ್ರ] ಸಾರ್ವಜನಿಕ ಶಿಕ್ಷಣ ಇಲಾಖೆಯ ಆಯುಕ್ತರ ಕಾರ್ಯಾಲಯ ಬೆಂಗಳೂರು ಇದರಡಿ ಕೆಳಕಂಡ ಕಾರ್ಯಲಯಗಳಲ್ಲಿ ಯೋಜನೇತರದಡಿ ಸೇವೆ

